CPMG / KA / BG-GPO/13/2003-2005 ಸುವರ್ಣ ಕರ್ನಾಟಕ 2006



# ಕರ್ನಾಟಕ ರಾಜ್ಯಪತ್ರ

ಅಧಿಕೃತವಾಗಿ ಪ್ರಕಟಿಸಲಾದುದು

ಸಂಪುಟ ೧೪೦ | ಬೆಂಗಳೂರು, ಗುರುವಾರ, ಸೆಪ್ಟೆಂಬರ್ ೨೯, ೨೦೦೬ (ಆಶ್ವಯುಜ ೮, ಶಕ ವರ್ಷ ೧೯೨೮) | ಸಂಚಿಕೆ ೩೯

## ಭಾಗ - ೩

## ಸರ್ಕಾರದ ಆಯಾ ಇಲಾಖೆಗಳ ಮುಖ್ಯಸ್ಥರ ಮತ್ತು ಸ್ಥಳೀಯ ಪ್ರಾಧಿಕಾರಿಗಳಿಗೆ ಸಂಬಂಧಿಸಿದ ಅಧಿಸೂಚನೆಗಳು

### ಸಹಕಾರ ಇಲಾಖೆ

**ಸಹಕಾರ ಸಂಘಗಳ ಸಹಾಯಕ ನಿಬಂಧಕರು, (ನಿ.441) ಹಾಗೂ ವಸೂಲಾಧಿಕಾರಿಗಳು,**

**ಕರ್ನಾಟಕ ರಾಜ್ಯ ಸಹಕಾರ ಪಟ್ಟಣ ಬ್ಯಾಂಕುಗಳ ಮಹಾಮಂಡಳ ನಿ., ಬೆಂಗಳೂರು ಇವರ ನಡವಳಿಕೆಗಳು**

**ವಿಷಯ:** ಸಿಂಧನೂರು ಅರ್ಬನ್ ಸೌಹಾರ್ದ ಕೋ-ಆಪರೇಟಿವ್ ಬ್ಯಾಂಕ್ ಲಿ., ಸಿಂಧನೂರು ಇದರ ಅಮಲ್ಜಾರಿ ಅರ್ಜಿ ಸಂಖ್ಯೆ:10/2004-05ಕ್ಕೆ ಸಂಬಂಧಪಟ್ಟಂತೆ ಸ್ಥಿರಾಸ್ತಿಯನ್ನು 1960ನೇ ಕರ್ನಾಟಕ ರಾಜ್ಯ ಸಹಕಾರ ಸಂಘಗಳ ನಿಯಮಗಳು, ನಿಯಮ 38 (7) (ಎ)ರ ಪ್ರಕಾರ ಮಾರಾಟ ಸ್ಥಿರೀಕರಣಗೊಳಿಸುವ ಬಗ್ಗೆ.

**ಉಲ್ಲೇಖ:**
1. ದಾವಾ ಸಂಖ್ಯೆ: 853/2003-04
2. ಅಮಲ್ಜಾರಿ ಅರ್ಜಿ ಸಂಖ್ಯೆ: 10/2004-05
3. ಮಾರಾಟಾಧಿಕಾರಿಯವರ ವರದಿ ದಿನಾಂಕ: 7.4.2005.

**ಪ್ರಸ್ತಾವನೆ:**

ಶ್ರೀ ಕೃಷ್ಣಯ್ಯ ಶೆಟ್ಟಿ ತಂ।। ಹನುಮಂತಯ್ಯ ಶೆಟ್ಟಿ ಸಾ।। ತುರ್ವಿಹಾಳ (ತಾ।। ಸಿಂಧನೂರು) ಇವರು ಸಿಂಧನೂರು ಅರ್ಬನ್ ಸೌಹಾರ್ದ ಕೋ-ಆಪರೇಟಿವ್ ಬ್ಯಾಂಕ್ ಲಿ., ಸಿಂಧನೂರು ಈ ಬ್ಯಾಂಕಿನಿಂದ ದಿನಾಂಕ:19.4.2001 ರಂದು ರೂ.60,000/- ಗಳನ್ನು (ಅರವತ್ತು ಸಾವಿರ ರೂಪಾಯಿಗಳು ಮಾತ್ರ) ಸಾಲವಾಗಿ ಪಡೆದು ಬ್ಯಾಂಕಿನ ಸಾಲ ಮಂಜೂರಾತಿಯ ಷರತ್ತು ಮತ್ತು ನಿಯಮಗಳ ಪ್ರಕಾರ ಸಾಲವನ್ನು ಮರುಪಾವತಿಸಲು ವಿಫಲರಾಗಿ ಸುಸ್ತಿದಾರರಾದ ಕಾರಣ ಸಾಲ ವಸೂಲಾತಿಗಾಗಿ ಕರ್ನಾಟಕ ಸಹಕಾರ ಸಂಘಗಳ ಕಾಯ್ದೆ 1959ರ ಕಲಂ 70ರನ್ವಯ ರಾಯಚೂರು ಜಿಲ್ಲಾ ಸಹಕಾರ ಸಂಘಗಳ ಗೌರವ ಮಧ್ಯಸ್ಥಿಕೆದಾರರು, ಸಿಂಧನೂರು ಇವರ ನ್ಯಾಯಾಲಯದಲ್ಲಿ ದಾವಾ ಸಂಖ್ಯೆ:853/2003-04 ರಂತೆ ದಾವಾ ಹೂಡಿ ಆದೇಶ ಪಡೆದಿದ್ದರೂ ಸಾಲದ ಬಾಕಿ ವಸೂಲಾತಿಯಾಗಿರುವುದಿಲ್ಲ.

ರಾಯಚೂರು ಜಿಲ್ಲಾ ಸಹಕಾರ ಸಂಘಗಳ ಗೌರವ ಮಧ್ಯಸ್ಥಿಕೆದಾರರು, ಸಿಂಧನೂರು ಇವರ ನ್ಯಾಯಾಲಯದಿಂದ ಪಡೆದ ಡಿಕ್ರಿ ಆದೇಶದನ್ವಯ ಸಿಂಧನೂರು ಅರ್ಬನ್ ಸೌಹಾರ್ದ ಕೋ-ಆಪರೇಟಿವ್ ಬ್ಯಾಂಕ್ ಲಿ., ಸಿಂಧನೂರು ಇದರ ಮುಖ್ಯ ಕಾರ್ಯನಿರ್ವಾಹಣಾಧಿಕಾರಿಯವರು, ಕರ್ನಾಟಕ ಸಹಕಾರ ಸಂಘಗಳ ನಿಯಮಗಳು 1960ರ ನಿಯಮ 34 (1)ರನ್ವಯ ಸಹಕಾರ ಸಂಘಗಳ ಸಹಾಯಕ ನಿಬಂಧಕರು, ಸಿಂಧನೂರು ಈ ಕಛೇರಿಯಲ್ಲಿ ಅಮಲ್ಜಾರಿ ಅರ್ಜಿ ಸಂಖ್ಯೆ:10/2004-05 ರಂತೆ ಕ್ರಮ ಕೈಗೊಳ್ಳಲು ದಾಖಲು ಮಾಡಲಾಗಿತ್ತು. ಸದರಿ ಅಮಲ್ಜಾರಿ ಅರ್ಜಿಯನ್ನು ಬ್ಯಾಂಕಿನ ಮಾರಾಟಾಧಿಕಾರಿಯವರಿಗೆ ವಹಿಸಲಾಗಿತ್ತು. ಸದರಿ ಮಾರಾಟಾಧಿಕಾರಿಯವರು ಅಂತಿಮವಾಗಿ ಅಮಲ್ಜಾರಿ ಕ್ರಮ ಕೈಗೊಂಡು ಸಾಲಕ್ಕೆ ಬ್ಯಾಂಕಿಗೆ ಆಧಾರ ಮಾಡಿದ್ದ ಈ ಕೆಳಗೆ ಕಾಣಿಸಿದ ಸ್ಥಿರಾಸ್ಥಿಯನ್ನು ದಿನಾಂಕ:21.3.2005 ರಂದು ಸಾರ್ವಜನಿಕ ಹರಾಜಿಗೆ ತರಲಾಗಿತ್ತು. ಸದರಿ ದಿನ ನಡೆಸಿದ ಹರಾಜಿನಲ್ಲಿ 3 ಜನ ಬಿಡ್ಡುದಾರರು ಭಾಗವಹಿಸಿದ್ದು, ಈ ಪೈಕಿ ಗುರುರಾಜ ಹೆಚ್. ಈ. ತಂ।। ವೆಂಕೋಬಯ್ಯಶೆಟ್ಟಿ ಸಾ।। ತುರ್ವಿಹಾಳ (ತಾ।। ಸಿಂಧನೂರು) ಇವರು ರೂ. 40,000/- ಗಳಿಗೆ (ನಲವತ್ತು ಸಾವಿರ ರೂಪಾಯಿಗಳು ಮಾತ್ರ) ಬಿಡ್ಡು ಮಾಡಿದ್ದು ಅತೀ ಹೆಚ್ಚಿನ ಬಿಡ್ಡುದಾರರಾಗಿರುತ್ತಾರೆ.

ಡಿಕ್ರಿ ಆದೇಶ ಮತ್ತು ಅಮಲ್ಜಾರಿ ಅರ್ಜಿಯನ್ವಯ ರೂ. 53,561/- ಗಳು (ಬಡ್ಡಿ ಮತ್ತು ಇತರೆ ವೆಚ್ಚಗಳು ಸೇರಿ) ಬ್ಯಾಂಕಿಗೆ ಬರಬೇಕಾಗಿರುತ್ತದೆ. ರೂ. 40,000/- ಗಳ ಅತೀ ಹೆಚ್ಚಿನ ಬಿಡ್ಡುದಾರರಾದ ಶ್ರೀ ಗುರುರಾಜ ಹೆಚ್.ಈ. ತಂ।. ವೆಂಕೋಬಯ್ಯಶೆಟ್ಟಿ ಸಾ।। ತುರ್ವಿಹಾಳ

(ತಾ।। ಸಿಂಧನೂರು) ಇವರು ಬಿಡ್ಡಿನ ಮೊತ್ತದ ಶೇಕಡಾ 15, ರೂ. 6000/- ಗಳನ್ನು ಹರಾಜಿನ ಸ್ಥಳದಲ್ಲಿಯೇ ಬ್ಯಾಂಕಿಗೆ ಪಾವತಿ ಮಾಡಿರುತ್ತಾರೆ. ಉಳಿಕೆ ಬಾಕಿ ಮೊತ್ತವನ್ನು ದಿನಾಂಕ 02.04.2005 ರಂದು ರೂ. 34,000/- ಗಳನ್ನು ಪಾವತಿಮಾಡಿರುತ್ತಾರೆ.

ಸಿಂಧನೂರು ಅರ್ಬನ್ ಸೌಹಾರ್ದ ಕೋ-ಆಪರೇಟಿವ್ ಬ್ಯಾಂಕ್ ಲಿ., ಸಿಂಧನೂರು ಇದರ ಮಾರಾಟಾಧಿಕಾರಿಯವರು ದಿನಾಂಕ:21.3.2005 ರಂದು ನಡೆಸಿದ ಸಾರ್ವಜನಿಕ ಹರಾಜನ್ನು ಕರ್ನಾಟಕ ಸಹಕಾರ ಸಂಘಗಳ ಕಾನೂನು ಮತ್ತು ನಿಯಮಗಳನ್ನು ಪಾಲಿಸಿ ಹರಾಜು ಕ್ರಮವನ್ನು ನಡೆಸಿರುವುದಾಗಿ, ಹಾಗೂ ಶ್ರೀ ಕೃಷ್ಣಯ್ಯ ಶೆಟ್ಟಿ ತಂ।। ಹನುಮಂತಯ್ಯ ಶೆಟ್ಟಿ ಸಾ।। ತುರ್ವಿಹಾಳ (ತಾ।। ಸಿಂಧನೂರು) ಇವರ ಸ್ಥಿರಾಸ್ತಿಯನ್ನು ಶ್ರೀ ಗುರುರಾಜ ಹೆಚ್. ಈ. ತಂ।। ವೆಂಕೋಬಯ್ಯಶೆಟ್ಟಿ ಸಾ।। ತುರ್ವಿಹಾಳ ಇವರಿಗೆ ಮಾರಾಟ ಮಾಡಿರುವ ಆಸ್ತಿಯ ಹರಾಜನ್ನು ಖಾಯಂಗೊಳಿಸಬೇಕೆಂದು ಉಲ್ಲೇಖ (3)ರಂತೆ ಈ ಕಛೇರಿಗೆ ಸವಿಸ್ತಾರವಾದ ವರದಿಯನ್ನು ಸಲ್ಲಿಸಿರುತ್ತಾರೆ.

ದಿನಾಂಕ: 21.3.2005ರಂದು ನಡೆಸಿದ ಸ್ಥಿರಾಸ್ತಿ ಬಹಿರಂಗ ಹರಾಜಿನ ನಡವಳಿಕೆಯನ್ನು ಪರಿಶೀಲಿಸಿದಾಗ ಸದರಿ ಸ್ಥಿರಾಸ್ತಿ ಬಹಿರಂಗ ಹರಾಜಿನಲ್ಲಿ ಒಟ್ಟು 3 ಜನ ಬಿಡ್ಡುದಾರರು ಭಾಗವಹಿಸಿದ್ದು, ಈ ಪೈಕಿ ಅತ್ಯಧಿಕ ಬಿಡ್ಡುದಾರರಾದ ಶ್ರೀ ಗುರುರಾಜ ಹೆಚ್.ಈ. ತಂ।। ವೆಂಕೋಬಯ್ಯಶೆಟ್ಟಿ ಸಾ।। ತುರ್ವಿಹಾಳ ಇವರಿಗೆ ರೂ. 40,000/- ಗಳಿಗೆ ಮಾರಾಟ ಮಾಡಿರುವುದು ದಾಖಲಾತಿಗಳಿಂದ ತಿಳಿದು ಬಂದಿರುತ್ತದೆ. ಬಹಿರಂಗ ಹರಾಜು ನಡೆದ 30 ದಿನಗಳೊಳಗೆ ಬಾಕಿದಾರರು ವಾದಿ ಬ್ಯಾಂಕಿಗೆ ಬರಬೇಕಾದ ಸಾಲವನ್ನು ಮರುಪಾವತಿ ಮಾಡದಿರುವುದರಿಂದ ಮತ್ತು ಈ ಬಗ್ಗೆ ಯಾವುದೇ ಆಕ್ಷೇಪಣೆ ಸಲ್ಲಿಸದೇ ಇರುವುದರಿಂದ ದಿನಾಂಕ:21.3.2005 ರಂದು ನಡೆಸಲಾದ ಸ್ಥಿರಾಸ್ತಿ ಹರಾಜನ್ನು ಖಾಯಂಗೊಳಿಸಬಹುದೆಂದು ಮಾರಾಟಾಧಿಕಾರಿಯವರು ಸಲ್ಲಿಸಿದ ವರದಿಯನ್ನು ಪರಿಶೀಲಿಸಿ ಮಾರಾಟಾಧಿಕಾರಿಯವರು ಕೈಗೊಂಡ ಕ್ರಮಗಳು ಕಾನೂನು ಬದ್ಧವಾಗಿದೆ ಎಂದು ಕಂಡು ಬಂದಿರುವುದರಿಂದ ಹಾಗೂ ಈ ಪೂರ್ಣ ಮಾರಾಟ ಪ್ರಕ್ರಿಯೆಯು ಕರ್ನಾಟಕ ಸಹಕಾರ ಸಂಘಗಳ ಕಾಯ್ದೆ 1959, ನಿಯಮಗಳು 1960ರ ಪ್ರಕಾರ ಜರುಗಿದ್ದು, ಮಾರಾಟ ಸ್ಥಿರೀಕರಣ ಸಮಯದಲ್ಲಿ ಕರ್ನಾಟಕ ರಾಜ್ಯ ಸೌಹಾರ್ದ ಸಹಕಾರಿ ಕಾಯ್ದೆ 1997, ನಿಯಮಗಳು 2004 ಹಾಲಿ ಜಾರಿಯಲ್ಲಿರುವ ಪ್ರಯುಕ್ತ ಈ ನಿಯಮಗಳ ಪ್ರಕಾರ ಈ ಕೆಳಗಿನ ಸ್ಥಿರೀಕರಣ ಆದೇಶ ಹೊರಡಿಸಲಾಗಿದೆ.

**ಆದೇಶ ಸಿ.ಇ.ಪಿ. ಸಂಖ್ಯೆ: ಎ.ಆರ್.ಇ/ಯು.ಬಿ.ಎಫ್/26/04-05 ದಿನಾಂಕ: 8ನೇ ಆಗಸ್ಟ್ 2005**

ಎಸ್.ಎಸ್. ಕಟಗೇರಿ, ಸಹಕಾರ ಸಂಘಗಳ ಸಹಾಯಕ ನಿಬಂಧಕರು (ನಿ-441) ಹಾಗೂ ವಸೂಲಾಧಿಕಾರಿಗಳು, ಕರ್ನಾಟಕ ರಾಜ್ಯ ಸಹಕಾರ ಪಟ್ಟಣ ಬ್ಯಾಂಕುಗಳ ಮಹಾಮಂಡಳ ನಿ., ಬೆಂಗಳೂರು ಆದ ನಾನು ಕರ್ನಾಟಕ ರಾಜ್ಯ ಸೌಹಾರ್ದ ಸಹಕಾರಿ ನಿಯಮಗಳು 2004ರ ನಿಯಮ 17(7)ರ ಪ್ರಕಾರ ದತ್ತವಾಗಿರುವ ಅಧಿಕಾರವನ್ನು ಉಪಯೋಗಿಸಿ ಅಮಲ್ಜಾರಿ ಅರ್ಜಿ ಸಂಖ್ಯೆ:10/2004-05ರಲ್ಲಿ ಶ್ರೀ ಕೃಷ್ಣಯ್ಯ ಶೆಟ್ಟಿ ತಂ।। ಹನುಮಂತಯ್ಯ ಶೆಟ್ಟಿ ಸಾ।। ತುರ್ವಿಹಾಳ (ತಾ।। ಸಿಂಧನೂರು) ಸದಸ್ಯತ್ವ ಸಂಖ್ಯೆ: ನಂ:1587 ಇವರಿಗೆ ಸೇರಿದ ಸ್ಥಿರಾಸ್ತಿಯನ್ನು ದಿನಾಂಕ:21.3.2005ರಂದು ವಾದಿ ಬ್ಯಾಂಕಿನ ಮಾರಾಟಾಧಿಕಾರಿಯವರು ಮಾಡಿದ ಬಹಿರಂಗ ಹರಾಜಿನಲ್ಲಿ ಶ್ರೀ ಗುರುರಾಜ ಹೆಚ್.ಈ. ತಂ।। ವೆಂಕೋಬಯ್ಯಶೆಟ್ಟಿ ಸಾ।। ತುರ್ವಿಹಾಳ ಇವರು ಅತೀ ಹೆಚ್ಚಿನ ಬಿಡ್ಡುದಾರರಾಗಿದ್ದು, ಇವರಿಗೆ ರೂ.40,000/- ಗಳಿಗೆ ಈ ಕೆಳಗೆ ವಿವರಿಸಿದ ಸ್ಥಿರಾಸ್ಥಿಯನ್ನು ಬಹಿರಂಗವಾಗಿ ಹರಾಜು ಮೂಲಕ ಮಾರಾಟ ಮಾಡಿರುವುದನ್ನು ಖಾಯಂಗೊಳಿಸಿ ಸ್ಥಿರೀಕರಿಸಿರುತ್ತೇನೆ.

**ಸ್ಥಿರಾಸ್ತಿಯ ವಿವರ**

ರಾಯಚೂರು ಜಿಲ್ಲೆ ಸಿಂಧನೂರು ತಾಲ್ಲೂಕಾ ಸಿಂಧನೂರು ಪಟ್ಟಣದಲ್ಲಿ ಕಾಲೇಜು ಹಿಂದುಗಡೆ, ಹಳ್ಳದ ದಂಡೆಗೆ ಇರುವ ಖಾಲಿ ನಿವೇಶನ ಸರ್ವೆ ನಂ. 964/ಬಿ, ಕ್ಷೇತ್ರ: 4-21 ಗುಂಟೆ, ಇದು ಎನ್.ಎ. ಆಗಿದ್ದು ಆರ್ಡರ್ ನಂ. ಎ.ಎಲ್.ಎನ್ : 107/85-86, ದಿನಾಂಕ 25.6.1986, ಇದರಲ್ಲಿಯ ಪ್ಲಾಟ್ ನಂ. ಬಿ-29, ವಿಸ್ತೀರ್ಣ 40 X 30 ಅಡಿಗಳು ಇದರ ಚಕ್ಕುಬಂದಿ.

| | | |
|---|---|---|
| ಪೂರ್ವಕ್ಕೆ | : | ಪ್ಲಾಟ್ ನಂ: ಬಿ-39 |
| ಪಶ್ಚಿಮಕ್ಕೆ | : | 30 ಅಡಿ ಅಗಲದ ರಸ್ತೆ |
| ಉತ್ತರಕ್ಕೆ | : | ಪ್ಲಾಟ್ ನಂ ಬಿ-28 |
| ದಕ್ಷಿಣಕ್ಕೆ | : | ಪ್ಲಾಟ್ ನಂ ಬಿ-30 |

ಮಾರಾಟದ ಮೊಬಲಗು ರೂ. 40,000/-

ಮಾರಾಟ ಮಾಡಿದ ದಿನಾಂಕ: 21.3.2005

ಈ ಆದೇಶವನ್ನು ನನ್ನ ಸಹಿ ಮತ್ತು ಕಛೇರಿಯ ಮೊಹರಿನೊಂದಿಗೆ ದಿನಾಂಕ: 8.8.2005 ರಂದು ನೀಡಲಾಗಿದೆ.

ಸಹಕಾರಿಗಳ ಸಹಾಯಕ ರಿಜಿಸ್ಟ್ರಾರ್ (ನಿ.441) ಹಾಗೂ ವಸೂಲಾಧಿಕಾರಿಗಳು

ಪಿ.ಆರ್. 1267 ಕ.ರಾ.ಸ.ಪ.ಬ್ಯಾಂಕುಗಳ ಮಹಾಮಂಡಳ ನಿ., ನಂ.132, ಕೆ.ಹೆಚ್. ರಸ್ತೆ, ಬೆಂಗಳೂರು-560 027.

**ಸಹಕಾರ ಇಲಾಖೆ**

**ಸಹಕಾರ ಸಂಘಗಳ ಸಹಾಯಕ ನಿಬಂಧಕರು, (ನಿ.441) ಹಾಗೂ ವಸೂಲಾಧಿಕಾರಿಗಳು,**
**ಕರ್ನಾಟಕ ರಾಜ್ಯ ಸಹಕಾರ ಪಟ್ಟಣ ಬ್ಯಾಂಕುಗಳ ಮಹಾಮಂಡಳ ನಿ., ಬೆಂಗಳೂರು ಇವರ ನಡವಳಿಕೆಗಳು**

**ವಿಷಯ:** ಸಿಂಧನೂರು ಅರ್ಬನ್ ಸೌಹಾರ್ದ ಕೋ-ಆಪರೇಟಿವ್ ಬ್ಯಾಂಕ್ ಲಿ., ಸಿಂಧನೂರು ಇದರ ಅಮಲ್ಜಾರಿ ಅರ್ಜಿ ಸಂಖ್ಯೆ:15/2003-04ಕ್ಕೆ ಸಂಬಂಧಪಟ್ಟಂತೆ ಸ್ಥಿರಾಸ್ತಿಯನ್ನು 1960ನೇ ಕರ್ನಾಟಕ ರಾಜ್ಯ ಸಹಕಾರ ಸಂಘಗಳ ನಿಯಮಗಳು, ನಿಯಮ 38 (7) (ಎ)ರ ಪ್ರಕಾರ ಮಾರಾಟ ಸ್ಥಿರೀಕರಣಗೊಳಿಸುವ ಬಗ್ಗೆ.

**ಉಲ್ಲೇಖ:**
1. ದಾವಾ ಸಂಖ್ಯೆ: 27/2002-03
2. ಅಮಲ್ಜಾರಿ ಅರ್ಜಿ ಸಂಖ್ಯೆ: 15/2003-04
3. ಮಾರಾಟಾಧಿಕಾರಿಯವರ ವರದಿ ದಿನಾಂಕ: 18.4.2005

**ಪ್ರಸ್ತಾವನೆ:**

ಮೆ।। ಹೋಟೆಲ್ ಗೋಕುಲ್, ಮಾ।। ರವೀಂದ್ರ ಹೆಚ್. ಶೆಟ್ಟಿ, ತಂ।। ಹಿರಿಯಣ್ಣ ಶೆಟ್ಟಿ, ಸಾ।। ಸಿಂಧನೂರು. ಇವರು ಸಿಂಧನೂರು ಅರ್ಬನ್ ಸೌಹಾರ್ದ ಕೋ-ಆಪರೇಟಿವ್ ಬ್ಯಾಂಕ್ ಲಿ., ಸಿಂಧನೂರು ಈ ಬ್ಯಾಂಕಿನಿಂದ ದಿನಾಂಕ:18.9.2000 ರಂದು ರೂ.5,00,000/- ಗಳನ್ನು

(ಐದು ಲಕ್ಷ ರೂಪಾಯಿಗಳು ಮಾತ್ರ) ಸಾಲವಾಗಿ ಪಡೆದು ಬ್ಯಾಂಕಿನ ಸಾಲ ಮಂಜೂರಾತಿಯ ಷರತ್ತು ಮತ್ತು ನಿಯಮಗಳ ಪ್ರಕಾರ ಸಾಲವನ್ನು ಮರುಪಾವತಿಸಲು ವಿಫಲರಾಗಿ ಸುಸ್ತಿದಾರರಾದ ಕಾರಣ ಸಾಲ ವಸೂಲಾತಿಗಾಗಿ ಕರ್ನಾಟಕ ಸಹಕಾರ ಸಂಘಗಳ ಕಾಯ್ದೆ 1959ರ ಕಲಂ 70ರನ್ವಯ ಸಹಕಾರ ಸಂಘಗಳ ಸಹಾಯಕ ನಿಬಂಧಕರು ರಾಯಚೂರು ಇವರ ನ್ಯಾಯಾಲಯದಲ್ಲಿ ದಾವಾ ಸಂಖ್ಯೆ:27/2002-03 ರಂತೆ ದಾವಾ ಹೂಡಿ ಆದೇಶ ಪಡೆದಿದ್ದರೂ ಸಾಲದ ಬಾಕಿ ವಸೂಲಾತಿಯಾಗಿರುವುದಿಲ್ಲ.

ಸಹಕಾರ ಸಂಘಗಳ ಸಹಾಯಕ ನಿಬಂಧಕರು ರಾಯಚೂರು ಇವರ ನ್ಯಾಯಾಲಯದಿಂದ ಪಡೆದ ಡಿಕ್ರಿ ಆದೇಶದನ್ವಯ ಸಿಂಧನೂರು ಅರ್ಬನ್ ಸೌಹಾರ್ದ ಕೋ-ಆಪರೇಟಿವ್ ಬ್ಯಾಂಕ್ ಲಿ., ಸಿಂಧನೂರು ಇದರ ಮುಖ್ಯ ಕಾರ್ಯನಿರ್ವಾಹಣಾಧಿಕಾರಿಯವರು, ಕರ್ನಾಟಕ ಸಹಕಾರ ಸಂಘಗಳ ನಿಯಮಗಳು 1960ರ ನಿಯಮ 34 (1) ರನ್ವಯ ಸಹಕಾರ ಸಂಘಗಳ ಸಹಾಯಕ ನಿಬಂಧಕರು, ಸಿಂಧನೂರು ಈ ಕಛೇರಿಯಲ್ಲಿ ಅಮಲ್ಜಾರಿ ಅರ್ಜಿ ಸಂಖ್ಯೆ:15/2003-04 ರಂತೆ ಕ್ರಮ ಕೈಗೊಳ್ಳಲು ದಾಖಲು ಮಾಡಲಾಗಿತ್ತು. ಸದರಿ ಅಮಲ್ಜಾರಿ ಅರ್ಜಿಯನ್ನು ಬ್ಯಾಂಕಿನ ಮಾರಾಟಾಧಿಕಾರಿಯವರಿಗೆ ವಹಿಸಲಾಗಿತ್ತು. ಸದರಿ ಮಾರಾಟಾಧಿಕಾರಿಯವರು ಅಂತಿಮವಾಗಿ ಅಮಲ್ಜಾರಿ ಕ್ರಮ ಕೈಗೊಂಡು ಸಾಲಕ್ಕೆ ಬ್ಯಾಂಕಿಗೆ ಆಧಾರ ಮಾಡಿದ್ದ ಈ ಕೆಳಗೆ ಕಾಣಿಸಿದ ಸ್ಥಿರಾಸ್ತಿಯನ್ನು ದಿನಾಂಕ:13.1.2004 ರಂದು ಸಾರ್ವಜನಿಕ ಹರಾಜಿಗೆ ತರಲಾಗಿತ್ತು. ಸದರಿ ದಿನ ನಡೆಸಿದ ಹರಾಜಿನಲ್ಲಿ 4 ಜನ ಬಿಡ್ಡುದಾರರು ಭಾಗವಹಿಸಿದ್ದು, ಈ ಪೈಕಿ ಶ್ರೀ ಮರಿಸ್ವಾಮಿ ಹಿರೇಮಠ ತಂ॥ ಚಂದ್ರಯ್ಯ ಹಿರೇಮಠ ಸಾ॥ ಸಿಂಧನೂರು ಇವರು ರೂ. 1,25,000/- ಗಳಿಗೆ (ಒಂದು ಲಕ್ಷ ಇಪ್ಪತ್ತೈದು ಸಾವಿರ ರೂಪಾಯಿಗಳು ಮಾತ್ರ) ಬಿಡ್ಡು ಮಾಡಿದ್ದು ಅತೀ ಹೆಚ್ಚಿನ ಬಿಡ್ಡುದಾರರಾಗಿರುತ್ತಾರೆ.

ಡಿಕ್ರಿ ಆದೇಶ ಮತ್ತು ಅಮಲ್ಜಾರಿ ಅರ್ಜಿಯನ್ವಯ ರೂ. 2,74,311/- ಗಳು (ಬಡ್ಡಿ ಮತ್ತು ಇತರೆ ವೆಚ್ಚಗಳು ಸೇರಿ) ಬ್ಯಾಂಕಿಗೆ ಬರಬೇಕಾಗಿರುತ್ತದೆ. ರೂ. 1,25,000/- ಗಳ ಅತೀ ಹೆಚ್ಚಿನ ಬಿಡ್ಡುದಾರರಾದ ಶ್ರೀ ಮರಿಸ್ವಾಮಿ ಹಿರೇಮಠ ತಂ॥ ಚಂದ್ರಯ್ಯ ಹಿರೇಮಠ ಸಾ॥ ಸಿಂಧನೂರು ಇವರು ಬಿಡ್ಡಿನ ಮೊತ್ತದ ಶೇಕಡಾ 15, ರೂ. 18,750/- ಗಳನ್ನು ಹರಾಜಿನ ಸ್ಥಳದಲ್ಲಿಯೇ ಬ್ಯಾಂಕಿಗೆ ಪಾವತಿ ಮಾಡಿರುತ್ತಾರೆ. ಉಳಿಕೆ ಬಾಕಿ ಮೊತ್ತವನ್ನು ದಿನಾಂಕ 25.1.2004 ರಂದು ರೂ. 1,06,250/- ಗಳನ್ನು ಪಾವತಿಮಾಡಿರುತ್ತಾರೆ.

ಸಿಂಧನೂರು ಅರ್ಬನ್ ಸೌಹಾರ್ದ ಕೋ-ಆಪರೇಟಿವ್ ಬ್ಯಾಂಕ್ ಲಿ., ಸಿಂಧನೂರು. ಇದರ ಮಾರಾಟಾಧಿಕಾರಿಯವರು ದಿನಾಂಕ:13.1.2004 ರಂದು ನಡೆಸಿದ ಸಾರ್ವಜನಿಕ ಹರಾಜನ್ನು ಕರ್ನಾಟಕ ಸಹಕಾರ ಸಂಘಗಳ ಕಾನೂನು ಮತ್ತು ನಿಯಮಗಳನ್ನು ಪಾಲಿಸಿ ಹರಾಜು ಕ್ರಮವನ್ನು ನಡೆಸಿರುವುದಾಗಿ, ಹಾಗೂ ಶ್ರೀ ರವೀಂದ್ರ ಹೆಚ್. ಶೆಟ್ಟಿ, ತಂ॥ ಹಿರಿಯಣ್ಣ ಶೆಟ್ಟಿ, ಸಾ॥ ಸಿಂಧನೂರು ಇವರ ಸ್ಥಿರಾಸ್ತಿಯನ್ನು ಶ್ರೀ ಮರಿಸ್ವಾಮಿ ಹಿರೇಮಠ ತಂ॥ ಚಂದ್ರಯ್ಯ ಹಿರೇಮಠ ಸಾ॥ ಸಿಂಧನೂರು ಇವರಿಗೆ ಮಾರಾಟ ಮಾಡಿರುವ ಆಸ್ತಿಯ ಹರಾಜನ್ನು ಖಾಯಂಗೊಳಿಸಬೇಕೆಂದು ಉಲ್ಲೇಖ (3)ರಂತೆ ಈ ಕಛೇರಿಗೆ ಸವಿಸ್ತಾರವಾದ ವರದಿಯನ್ನು ಸಲ್ಲಿಸಿರುತ್ತಾರೆ.

ದಿನಾಂಕ: 13.1.2004ರಂದು ನಡೆಸಿದ ಸ್ಥಿರಾಸ್ತಿ ಬಹಿರಂಗ ಹರಾಜಿನ ನಡವಳಿಕೆಯನ್ನು ಪರಿಶೀಲಿಸಿದಾಗ ಸದರಿ ಸ್ಥಿರಾಸ್ತಿ ಬಹಿರಂಗ ಹರಾಜಿನಲ್ಲಿ ಒಟ್ಟು 3 ಜನ ಬಿಡ್ಡುದಾರರು ಭಾಗವಹಿಸಿದ್ದು, ಈ ಪೈಕಿ ಅತ್ಯಧಿಕ ಬಿಡ್ಡುದಾರರಾದ ಶ್ರೀ ಮರಿಸ್ವಾಮಿ ಹಿರೇಮಠ ತಂ॥ ಚಂದ್ರಯ್ಯ ಹಿರೇಮಠ ಸಾ॥ ಸಿಂಧನೂರು ಇವರಿಗೆ ರೂ. 1,25,000/- ಗಳಿಗೆ ಮಾರಾಟ ಮಾಡಿರುವುದು ದಾಖಲಾತಿಗಳಿಂದ ತಿಳಿದು ಬಂದಿರುತ್ತದೆ. ಬಹಿರಂಗ ಹರಾಜು ನಡೆದ 30 ದಿನಗಳೊಳಗೆ ಬಾಕಿದಾರರು ವಾದಿ ಬ್ಯಾಂಕಿಗೆ ಬರಬೇಕಾದ ಸಾಲವನ್ನು ಮರುಪಾವತಿ ಮಾಡದಿರುವುದರಿಂದ ಮತ್ತು ಈ ಬಗ್ಗೆ ಯಾವುದೇ ಆಕ್ಷೇಪಣೆ ಸಲ್ಲಿಸದೇ ಇರುವುದರಿಂದ ದಿನಾಂಕ:13.1.2004 ರಂದು ನಡೆಸಲಾದ ಸ್ಥಿರಾಸ್ತಿ ಹರಾಜನ್ನು ಖಾಯಂಗೊಳಿಸಬಹುದೆಂದು ಮಾರಾಟಾಧಿಕಾರಿಯವರು ಸಲ್ಲಿಸಿದ ವರದಿಯನ್ನು ಪರಿಶೀಲಿಸಿ ಮಾರಾಟಾಧಿಕಾರಿಯವರು ಕೈಗೊಂಡ ಕ್ರಮಗಳು ಕಾನೂನು ಬದ್ಧವಾಗಿದೆ ಎಂದು ಕಂಡು ಬಂದಿರುವುದರಿಂದ ಹಾಗೂ ಈ ಪೂರ್ಣ ಮಾರಾಟ ಪ್ರಕ್ರಿಯೆಯು ಕರ್ನಾಟಕ ಸಹಕಾರ ಸಂಘಗಳ ಕಾಯ್ದೆ 1959, ನಿಯಮಗಳು 1960ರ ಪ್ರಕಾರ ಜರುಗಿದ್ದು, ಮಾರಾಟ ಸ್ಥಿರೀಕರಣ ಸಮಯದಲ್ಲಿ ಕರ್ನಾಟಕ ರಾಜ್ಯ ಸೌಹಾರ್ದ ಸಹಕಾರಿ ಕಾಯ್ದೆ 1997, ನಿಯಮಗಳು 2004 ಹಾಲಿ ಜಾರಿಯಲ್ಲಿರುವ ಪ್ರಯುಕ್ತ ಈ ನಿಯಮಗಳ ಪ್ರಕಾರ ಈ ಕೆಳಗಿನ ಸ್ಥಿರೀಕರಣ ಆದೇಶ ಹೊರಡಿಸಲಾಗಿದೆ.

**ಆದೇಶ ಸಿ.ಇ.ಪಿ. ಸಂಖ್ಯೆ: ಎ.ಆರ್.ಇ/ಯು.ಬಿ.ಎಫ್/275/05-06 ದಿನಾಂಕ: 8ನೇ ಆಗಸ್ಟ್ 2005**

ಎಸ್.ಎಸ್. ಕಟಗೇರಿ, ಸಹಕಾರ ಸಂಘಗಳ ಸಹಾಯಕ ನಿಬಂಧಕರು (ನಿ-441) ಹಾಗೂ ವಸೂಲಾಧಿಕಾರಿಗಳು, ಕರ್ನಾಟಕ ರಾಜ್ಯ ಸಹಕಾರ ಪಟ್ಟಣ ಬ್ಯಾಂಕುಗಳ ಮಹಾಮಂಡಳ ನಿ., ಬೆಂಗಳೂರು ಆದ ನಾನು ಕರ್ನಾಟಕ ರಾಜ್ಯ ಸೌಹಾರ್ದ ಸಹಕಾರಿ ನಿಯಮಗಳು 2004ರ ನಿಯಮ 17(7)ರ ಪ್ರಕಾರ ದತ್ತವಾಗಿರುವ ಅಧಿಕಾರವನ್ನು ಉಪಯೋಗಿಸಿ ಅಮಲ್ಜಾರಿ ಅರ್ಜಿ ಸಂಖ್ಯೆ:15/2003-04ರಲ್ಲಿ ಮೆ॥ ಹೋಟೆಲ್ ಗೋಕುಲ್, ಮಾ॥ ರವೀಂದ್ರ ಹೆಚ್. ಶೆಟ್ಟಿ, ತಂ॥ ಹಿರಿಯಣ್ಣ ಶೆಟ್ಟಿ, ಸಾ॥ ಸಿಂಧನೂರು ಸದಸ್ಯತ್ವ ಸಂಖ್ಯೆ: ನಂ:1204 ಇವರಿಗೆ ಸೇರಿದ ಸ್ಥಿರಾಸ್ತಿಯನ್ನು ದಿನಾಂಕ:13.1.2004ರಂದು ವಾದಿ ಬ್ಯಾಂಕಿನ ಮಾರಾಟಾಧಿಕಾರಿಯವರು ಮಾಡಿದ ಬಹಿರಂಗ ಹರಾಜಿನಲ್ಲಿ ಶ್ರೀ ಮರಿಸ್ವಾಮಿ ಹಿರೇಮಠ ತಂ॥ ಚಂದ್ರಯ್ಯ ಹಿರೇಮಠ ಸಾ॥ ಸಿಂಧನೂರು ಇವರು ಅತೀ ಹೆಚ್ಚಿನ ಬಿಡ್ಡುದಾರರಾಗಿದ್ದು, ಇವರಿಗೆ ರೂ.1,25,000/- ಗಳಿಗೆ ಈ ಕೆಳಗೆ ವಿವರಿಸಿದ ಸ್ಥಿರಾಸ್ಥಿಯನ್ನು ಬಹಿರಂಗವಾಗಿ ಹರಾಜು ಮೂಲಕ ಮಾರಾಟ ಮಾಡಿರುವುದನ್ನು ಖಾಯಂಗೊಳಿಸಿ ಸ್ಥಿರೀಕರಿಸಿರುತ್ತೇನೆ.

**ಸ್ಥಿರಾಸ್ತಿಯ ವಿವರ**

ರಾಯಚೂರು ಜಿಲ್ಲೆ ಸಿಂಧನೂರು ಪಟ್ಟಣದ ಆದರ್ಶ ಕಾಲೋನಿಯಲ್ಲಿರುವ ಖಾಲಿ ನಿವೇಶನ ಸರ್ವೆ ನಂ. 777/1 ಎನ್.ಎ. ಆರ್ಡರ್ ನಂ. ಎ.ಎಲ್.ಎನ್. 23/87-88, ದಿನಾಂಕ 19.8.87, ಪ್ಲಾಟ್ ನಂ. 109, ಟಿ.ಎಂ.ಸಿ. ನಂ. 6-1-471/ಎ/109, ವಿಸ್ತೀರ್ಣ 30 x 60 ಅಡಿಗಳು ಇದರ ಚಕ್ಕುಬಂದಿ.

| | | |
|---|---|---|
| ಪೂರ್ವಕ್ಕೆ | : | 30 ಅಡಿ ರಸ್ತೆ, |
| ಪಶ್ಚಿಮಕ್ಕೆ | : | ಪ್ಲಾಟ್ ನಂ. 110 |
| ಉತ್ತರಕ್ಕೆ | : | 30 ಅಡಿ ರಸ್ತೆ, |
| ದಕ್ಷಿಣಕ್ಕೆ | : | ಬಸವರಾಜರ ಭೂಮಿ |

ಮಾರಾಟದ ಮೊಬಲಗು ರೂ. 1,25,000/-

ಮಾರಾಟ ಮಾಡಿದ ದಿನಾಂಕ: 13.1.2004

ಈ ಆದೇಶವನ್ನು ನನ್ನ ಸಹಿ ಮತ್ತು ಕಛೇರಿಯ ಮೊಹರಿನೊಂದಿಗೆ ದಿನಾಂಕ: 8.8.2005 ರಂದು ನೀಡಲಾಗಿದೆ.

ಸಹಕಾರಿಗಳ ಸಹಾಯಕ ರಿಜಿಸ್ಟ್ರಾರ್ (ನಿ.441) ಹಾಗೂ ವಸೂಲಾಧಿಕಾರಿಗಳು
ಕ.ರಾ.ಸ.ಪ.ಬ್ಯಾಂಕುಗಳ ಮಹಾಮಂಡಳ ನಿ., ನಂ.132, ಕೆ.ಹೆಚ್. ರಸ್ತೆ, ಬೆಂಗಳೂರು-560 027.

ಪಿ.ಆರ್. 1268

## ಸಹಕಾರ ಇಲಾಖೆ

### ಸಹಕಾರ ಸಂಘಗಳ ಸಹಾಯಕ ನಿಬಂಧಕರು, (ನಿ.441) ಹಾಗೂ ವಸೂಲಾಧಿಕಾರಿಗಳು, ಕರ್ನಾಟಕ ರಾಜ್ಯ ಸಹಕಾರ ಪಟ್ಟಣ ಬ್ಯಾಂಕುಗಳ ಮಹಾಮಂಡಳ ನಿ., ಬೆಂಗಳೂರು ಇವರ ನಡವಳಿಕೆಗಳು

**ವಿಷಯ:** ಸಿಂಧನೂರು ಅರ್ಬನ್ ಸೌಹಾರ್ದ ಕೋ-ಆಪರೇಟಿವ್ ಬ್ಯಾಂಕ್ ಲಿ., ಸಿಂಧನೂರು ಇದರ ಅಮಲ್ಜಾರಿ ಅರ್ಜಿ ಸಂಖ್ಯೆ:02/2003-04ಕ್ಕೆ ಸಂಬಂಧಪಟ್ಟಂತೆ ಸ್ಥಿರಾಸ್ತಿಯನ್ನು 1960ನೇ ಕರ್ನಾಟಕ ರಾಜ್ಯ ಸಹಕಾರ ಸಂಘಗಳ ನಿಯಮಗಳು, ನಿಯಮ 38 (7) (ಎ)ರ ಪ್ರಕಾರ ಮಾರಾಟ ಸ್ಥಿರೀಕರಣಗೊಳಿಸುವ ಬಗ್ಗೆ.

**ಉಲ್ಲೇಖ:**
1. ದಾವಾ ಸಂಖ್ಯೆ: 32/2002-03
2. ಅಮಲ್ಜಾರಿ ಅರ್ಜಿ ಸಂಖ್ಯೆ: 02/2003-04
3. ಮಾರಾಟಾಧಿಕಾರಿಯವರ ವರದಿ ದಿನಾಂಕ: 7.4.2005

**ಪ್ರಸ್ತಾವನೆ:**

ಶ್ರೀ ಪ್ರಭಾಕರ ರಾವ್ ಕೆ. ತಂ|| ವೆಂಕಟರಾವ ಸಾ|| ಮುಚ್ಚಳಕ್ಯಾಂಪ (ತಾ|| ಸಿಂಧನೂರು) ಇವರು ಸಿಂಧನೂರು ಅರ್ಬನ್ ಸೌಹಾರ್ದ ಕೋ-ಆಪರೇಟಿವ್ ಬ್ಯಾಂಕ್ ಲಿ., ಸಿಂಧನೂರು ಈ ಬ್ಯಾಂಕಿನಿಂದ ದಿನಾಂಕ:10.4.2000 ರಂದು ರೂ.3,76,000/- ಗಳನ್ನು (ಮೂರುಲಕ್ಷ ಎಪ್ಪತ್ತಾರು ಸಾವಿರ ರೂಪಾಯಿಗಳು ಮಾತ್ರ) ಸಾಲವಾಗಿ ಪಡೆದು ಬ್ಯಾಂಕಿನ ಸಾಲ ಮಂಜೂರಾತಿಯ ಷರತ್ತು ಮತ್ತು ನಿಯಮಗಳ ಪ್ರಕಾರ ಸಾಲವನ್ನು ಮರುಪಾವತಿಸಲು ವಿಫಲರಾಗಿ ಸುಸ್ತಿದಾರರಾದ ಕಾರಣ ಸಾಲ ವಸೂಲಾತಿಗಾಗಿ ಕರ್ನಾಟಕ ಸಹಕಾರ ಸಂಘಗಳ ಕಾಯ್ದೆ 1959ರ ಕಲಂ 70ರನ್ವಯ ಸಹಕಾರಿಗಳ ಸಹಾಯಕ ನಿಬಂಧಕರು ರಾಯಚೂರು ಇವರ ನ್ಯಾಯಾಲಯದಲ್ಲಿ ದಾವಾ ಸಂಖ್ಯೆ:32/2002-03 ರಂತೆ ದಾವಾ ಹೂಡಿ ಆದೇಶ ಪಡೆದಿದ್ದರೂ ಸಾಲದ ಬಾಕಿ ವಸೂಲಾತಿಯಾಗಿರುವುದಿಲ್ಲ.

ಸಹಕಾರಿಗಳ ಸಹಾಯಕ ನಿಬಂಧಕರು ರಾಯಚೂರು ಇವರ ನ್ಯಾಯಾಲಯದಿಂದ ಪಡೆದ ಡಿಕ್ರಿ ಆದೇಶದನ್ವಯ ಸಿಂಧನೂರು ಅರ್ಬನ್ ಸೌಹಾರ್ದ ಕೋ-ಆಪರೇಟಿವ್ ಬ್ಯಾಂಕ್ ಲಿ., ಸಿಂಧನೂರು ಇದರ ಮುಖ್ಯ ಕಾರ್ಯನಿರ್ವಾಹಣಾಧಿಕಾರಿಯವರು, ಕರ್ನಾಟಕ ಸಹಕಾರ ಸಂಘಗಳ ನಿಯಮಗಳು 1960ರ ನಿಯಮ 34 (1) ರನ್ವಯ ಸಹಕಾರ ಸಂಘಗಳ ಸಹಾಯಕ ನಿಬಂಧಕರು, ಸಿಂಧನೂರು ಈ ಕಛೇರಿಯಲ್ಲಿ ಅಮಲ್ಜಾರಿ ಅರ್ಜಿ ಸಂಖ್ಯೆ:02/2003-04 ರಂತೆ ಕ್ರಮ ಕೈಗೊಳ್ಳಲು ದಾಖಲು ಮಾಡಲಾಗಿತ್ತು. ಸದರಿ ಅಮಲ್ಜಾರಿ ಅರ್ಜಿಯನ್ನು ಬ್ಯಾಂಕಿನ ಮಾರಾಟಾಧಿಕಾರಿಯವರಿಗೆ ವಹಿಸಲಾಗಿತ್ತು. ಸದರಿ ಮಾರಾಟಾಧಿಕಾರಿಯವರು ಅಂತಿಮವಾಗಿ ಅಮಲ್ಜಾರಿ ಕ್ರಮ ಕೈಗೊಂಡು ಸಾಲಕ್ಕೆ ಬ್ಯಾಂಕಿಗೆ ಆಧಾರ ಮಾಡಿದ್ದ ಈ ಕೆಳಗೆ ಕಾಣಿಸಿದ ಸ್ಥಿರಾಸ್ತಿಯನ್ನು ದಿನಾಂಕ:21.3.2005 ರಂದು ಸಾರ್ವಜನಿಕ ಹರಾಜಿಗೆ ತರಲಾಗಿತ್ತು. ಸದರಿ ದಿನ ನಡೆಸಿದ ಹರಾಜಿನಲ್ಲಿ 3 ಜನ ಬಿಡ್ಡುದಾರರು ಭಾಗವಹಿಸಿದ್ದು, ಈ ಪೈಕಿ ಶ್ರೀಮತಿ ಕಲಾವತಿ ಗಂ|| ಗಜಾನನ ಸಾ|| ಸಿಂಧನೂರು ಇವರು ರೂ. 3,86,000/- ಗಳಿಗೆ (ಮೂರು ಲಕ್ಷ ಎಂಬತ್ತಾರು ಸಾವಿರ ರೂಪಾಯಿಗಳು ಮಾತ್ರ) ಬಿಡ್ಡು ಮಾಡಿದ್ದು ಅತೀ ಹೆಚ್ಚಿನ ಬಿಡ್ಡುದಾರರಾಗಿರುತ್ತಾರೆ.

ಡಿಕ್ರಿ ಆದೇಶ ಮತ್ತು ಅಮಲ್ಜಾರಿ ಅರ್ಜಿಯನ್ವಯ ರೂ. 2,83,605/- ಗಳು (ಬಡ್ಡಿ ಮತ್ತು ಇತರೆ ವೆಚ್ಚಗಳು ಸೇರಿ) ಬ್ಯಾಂಕಿಗೆ ಬರಬೇಕಾಗಿರುತ್ತದೆ. ರೂ. 3,86,000/- ಗಳ ಅತೀ ಹೆಚ್ಚಿನ ಬಿಡ್ಡುದಾರರಾದ ಶ್ರೀಮತಿ ಕಲಾವತಿ ಗಂ|| ಗಜಾನನ ಸಾ|| ಸಿಂಧನೂರು ಇವರು ಬಿಡ್ಡಿನ ಮೊತ್ತದ ಶೇಕಡಾ 15, ರೂ. 57,900/- ಗಳನ್ನು ಹರಾಜಿನ ಸ್ಥಳದಲ್ಲಿಯೇ ಬ್ಯಾಂಕಿಗೆ ಪಾವತಿ ಮಾಡಿರುತ್ತಾರೆ. ಉಳಿಕೆ ಬಾಕಿ ಮೊತ್ತವನ್ನು ದಿನಾಂಕ 2.4.2005 ರಂದು ರೂ. 3,28,100/- ಗಳನ್ನು ಪಾವತಿಮಾಡಿರುತ್ತಾರೆ.

ಸಿಂಧನೂರು ಅರ್ಬನ್ ಸೌಹಾರ್ದ ಕೋ-ಆಪರೇಟಿವ್ ಬ್ಯಾಂಕ್ ಲಿ., ಸಿಂಧನೂರು ಸಹಕಾರ ಇದರ ಮಾರಾಟಾಧಿಕಾರಿಯವರು ದಿನಾಂಕ:21.3.2005 ರಂದು ನಡೆಸಿದ ಸಾರ್ವಜನಿಕ ಹರಾಜನ್ನು ಕರ್ನಾಟಕ ಸಹಕಾರ ಸಂಘಗಳ ಕಾನೂನು ಮತ್ತು ನಿಯಮಗಳನ್ನು ಪಾಲಿಸಿ ಹರಾಜು ಕ್ರಮವನ್ನು ನಡೆಸಿರುವುದಾಗಿ, ಹಾಗೂ ಶ್ರೀ ಪ್ರಭಾಕರ ರಾವ್ ಕೆ. ತಂ|| ವೆಂಕಟರಾವ್ ಸಾ|| ಮುಚ್ಚಳಕ್ಯಾಂಪ ಮತ್ತು ಶ್ರೀ ರಾಮಾರಾವ ಕೆ. ತಂ|| ವೆಂಕಟರಾವ ಸಾ|| ಮುಚ್ಚಳಕ್ಯಾಂಪ (ತಾ|| ಸಿಂಧನೂರು) ಇವರ ಸ್ಥಿರಾಸ್ತಿಯನ್ನು ಶ್ರೀಮತಿ ಕಲಾವತಿ ಗಂ|| ಗಜಾನನ ಸಾ|| ಸಿಂಧನೂರು ಇವರಿಗೆ ಮಾರಾಟ ಮಾಡಿರುವ ಆಸ್ತಿಯ ಹರಾಜನ್ನು ಖಾಯಂಗೊಳಿಸಬೇಕೆಂದು ಉಲ್ಲೇಖ (3)ರಂತೆ ಈ ಕಛೇರಿಗೆ ಸವಿಸ್ತಾರವಾದ ವರದಿಯನ್ನು ಸಲ್ಲಿಸಿರುತ್ತಾರೆ.

ದಿನಾಂಕ: 21.3.2005ರಂದು ನಡೆಸಿದ ಸ್ಥಿರಾಸ್ತಿ ಬಹಿರಂಗ ಹರಾಜಿನ ನಡವಳಿಕೆಯನ್ನು ಪರಿಶೀಲಿಸಿದಾಗ ಸದರಿ ಸ್ಥಿರಾಸ್ತಿ ಬಹಿರಂಗ ಹರಾಜಿನಲ್ಲಿ ಒಟ್ಟು 3 ಜನ ಬಿಡ್ಡುದಾರರು ಭಾಗವಹಿಸಿದ್ದು, ಈ ಪೈಕಿ ಅತ್ಯಧಿಕ ಬಿಡ್ಡುದಾರರಾದ ಶ್ರೀಮತಿ ಕಲಾವತಿ ಗಂ|| ಗಜಾನನ ಸಾ|| ಸಿಂಧನೂರು ಇವರಿಗೆ ರೂ. 3,86,000/- ಗಳಿಗೆ ಮಾರಾಟ ಮಾಡಿರುವುದು ದಾಖಲಾತಿಗಳಿಂದ ತಿಳಿದು ಬಂದಿರುತ್ತದೆ. ಬಹಿರಂಗ ಹರಾಜು ನಡೆದ 30 ದಿನಗಳೊಳಗೆ ಬಾಕಿದಾರರು ವಾದಿ ಬ್ಯಾಂಕಿಗೆ ಬರಬೇಕಾದ ಸಾಲವನ್ನು ಮರುಪಾವತಿ ಮಾಡದಿರುವುದರಿಂದ ಮತ್ತು ಈ ಬಗ್ಗೆ ಯಾವುದೇ ಆಕ್ಷೇಪಣೆ ಸಲ್ಲಿಸದೇ ಇರುವುದರಿಂದ ದಿನಾಂಕ:21.3.2005 ರಂದು ನಡೆಸಲಾದ ಸ್ಥಿರಾಸ್ತಿ ಹರಾಜನ್ನು ಖಾಯಂಗೊಳಿಸಬಹುದೆಂದು ಮಾರಾಟಾಧಿಕಾರಿಯವರು ಸಲ್ಲಿಸಿದ ವರದಿಯನ್ನು ಪರಿಶೀಲಿಸಿ ಮಾರಾಟಾಧಿಕಾರಿಯವರು ಕೈಗೊಂಡ ಕ್ರಮಗಳು ಕಾನೂನು ಬದ್ಧವಾಗಿದೆ ಎಂದು ಕಂಡು ಬಂದಿರುವುದರಿಂದ ಹಾಗೂ ಈ ಪೂರ್ಣ ಮಾರಾಟ ಪ್ರಕ್ರಿಯೆಯು ಕರ್ನಾಟಕ ಸಹಕಾರ ಸಂಘಗಳ ಕಾಯ್ದೆ 1959, ನಿಯಮಗಳು 1960ರ ಪ್ರಕಾರ ಜರುಗಿದ್ದು, ಮಾರಾಟ ಸ್ಥಿರೀಕರಣ ಸಮಯದಲ್ಲಿ ಕರ್ನಾಟಕ ರಾಜ್ಯ ಸೌಹಾರ್ದ ಸಹಕಾರಿ ಕಾಯ್ದೆ 1997, ನಿಯಮಗಳು 2004 ಹಾಲಿ ಜಾರಿಯಲ್ಲಿರುವ ಪ್ರಯುಕ್ತ ಈ ನಿಯಮಗಳ ಪ್ರಕಾರ ಈ ಕೆಳಗಿನ ಸ್ಥಿರೀಕರಣ ಆದೇಶ ಹೊರಡಿಸಲಾಗಿದೆ.

**ಆದೇಶ ಸಿ.ಇ.ಪಿ. ಸಂಖ್ಯೆ: ಎ.ಆರ್.ಇ/ಯು.ಬಿ.ಎಫ್/03/04-05 ದಿನಾಂಕ: 8ನೇ ಆಗಸ್ಟ್ 2005**

ಎಸ್.ಎಸ್. ಕಟಗೇರಿ, ಸಹಕಾರ ಸಂಘಗಳ ಸಹಾಯಕ ನಿಬಂಧಕರು (ನಿ-441) ಹಾಗೂ ವಸೂಲಾಧಿಕಾರಿಗಳು, ಕರ್ನಾಟಕ ರಾಜ್ಯ ಸಹಕಾರ ಪಟ್ಟಣ ಬ್ಯಾಂಕುಗಳ ಮಹಾಮಂಡಳ ನಿ., ಬೆಂಗಳೂರು ಆದ ನಾನು ಕರ್ನಾಟಕ ರಾಜ್ಯ ಸೌಹಾರ್ದ ಸಹಕಾರಿ ನಿಯಮಗಳು 2004ರ ನಿಯಮ 17(7)ರ ಪ್ರಕಾರ ದತ್ತವಾಗಿರುವ ಅಧಿಕಾರವನ್ನು ಉಪಯೋಗಿಸಿ ಅಮಲ್ಜಾರಿ ಅರ್ಜಿ ಸಂಖ್ಯೆ:02/2003-04ರಲ್ಲಿ ಶ್ರೀ ಪ್ರಭಾಕರ ರಾವ ಕೆ. ತಂ|| ವೆಂಕಟರಾವ ಸಾ|| ಮುಚ್ಚಳಕ್ಯಾಂಪ (ತಾ|| ಸಿಂಧನೂರು) ಸದಸ್ಯತ್ವ ಸಂಖ್ಯೆ: ನಂ:574 ಇವರಿಗೆ ಭದ್ರತೆಯಾಗಿ ನೀಡಿರುವ ಶ್ರೀ ಪ್ರಭಾಕರ ರಾವ ಕೆ. ತಂ|| ವೆಂಕಟರಾವ ಸಾ|| ಮುಚ್ಚಳಕ್ಯಾಂಪ ಮತ್ತು ಶ್ರೀ ರಾಮರಾವ ಕೆ. ತಂ|| ವೆಂಕಟರಾವ ಸಾ|| ಮುಚ್ಚಳಕ್ಯಾಂಪ (ತಾ|| ಸಿಂಧನೂರು) ಇವರಿಗೆ ಸೇರಿದ ಸ್ಥಿರಾಸ್ತಿಯನ್ನು ದಿನಾಂಕ:21.3.2005ರಂದು ವಾದಿ ಬ್ಯಾಂಕಿನ ಮಾರಾಟಾಧಿಕಾರಿಯವರು ಮಾಡಿದ ಬಹಿರಂಗ ಹರಾಜಿನಲ್ಲಿ ಶ್ರೀಮತಿ ಕಲಾವತಿ ಗಂ|| ಗಜಾನನ ಸಾ||

ಸಿಂಧನೂರು ಇವರು ಅತೀ ಹೆಚ್ಚಿನ ಬಿಡ್ಡುದಾರರಾಗಿದ್ದು, ಇವರಿಗೆ ರೂ.3,86,000/- ಗಳಿಗೆ ಈ ಕೆಳಗೆ ವಿವರಿಸಿದ ಸ್ಥಿರಾಸ್ಥಿಯನ್ನು ಬಹಿರಂಗವಾಗಿ ಹರಾಜು ಮೂಲಕ ಮಾರಾಟ ಮಾಡಿರುವುದನ್ನು ಖಾಯಂಗೊಳಿಸಿ ಸ್ಥಿರೀಕರಿಸಿರುತ್ತೇನೆ.

**ಸ್ಥಿರಾಸ್ತಿಯ ವಿವರ**

ರಾಯಚೂರು ಜಿಲ್ಲೆ ಸಿಂಧನೂರು ತಾಲ್ಲೂಕಾ ಸಿಂಧನೂರು ಸೀಮಾದಲ್ಲಿ ಬರುವ ಮುಚ್ಚಳಕ್ಯಾಂಪ ಗ್ರಾಮದ ಸರ್ವೆ ನಂ. 326/ಕೆ, ವಿಸ್ತೀರ್ಣ 7 ಎಕರೆ 08 ಗುಂಟೆ ವ್ಯವಸಾಯ ಭೂಮಿ ಇದರ ಚಕ್ಕುಬಂದಿ

ಪೂರ್ವಕ್ಕೆ : ವ್ಯವಸಾಯ ಭೂಮಿ
ಪಶ್ಚಿಮಕ್ಕೆ : ವ್ಯವಸಾಯ ಭೂಮಿ
ಉತ್ತರಕ್ಕೆ : ವ್ಯವಸಾಯ ಭೂಮಿ
ದಕ್ಷಿಣಕ್ಕೆ : ರಸ್ತೆ

ಮಾರಾಟದ ಮೊಬಲಗು ರೂ. 3,86,000/-

ಮಾರಾಟ ಮಾಡಿದ ದಿನಾಂಕ: 21.3.2005

ಈ ಆದೇಶವನ್ನು ನನ್ನ ಸಹಿ ಮತ್ತು ಕಛೇರಿಯ ಮೊಹರಿನೊಂದಿಗೆ ದಿನಾಂಕ: 8.8.2005 ರಂದು ನೀಡಲಾಗಿದೆ.

ಸಹಕಾರಿಗಳ ಸಹಾಯಕ ರಿಜಿಸ್ಟಾರ್ (ನಿ.441) ಹಾಗೂ ವಸೂಲಾಧಿಕಾರಿಗಳು

ಪಿ.ಆರ್. 1269 ಕ.ರಾ.ಸ.ಪ.ಬ್ಯಾಂಕುಗಳ ಮಹಾಮಂಡಳ ನಿ., ನಂ.132, ಕೆ.ಹೆಚ್. ರಸ್ತೆ, ಬೆಂಗಳೂರು-560 027.

## ಸಹಕಾರ ಸಂಘಗಳ ಉಪ ನಿಬಂಧಕರ ಕಛೇರಿ, ಬೀದರ್ ಜಿಲ್ಲೆ, ಬೀದರ್

**ವಿಷಯ:** ಸಮಾಪನೆಗೊಂಡ ಹಾಲು ಉತ್ಪಾದಕರ ಸಹಕಾರ ಸಂಘ ನಿ, ಹಾರಕೂಡ ತಾ: ಬಸವಕಲ್ಯಾಣ ಇದರ ನೊಂದಣಿ ಸಂಖ್ಯೆ ರದ್ದುಪಡಿಸುವ ಕುರಿತು.

**ಉಲ್ಲೇಖ:**
1. ಈ ಕಛೇರಿ ಆದೇಶ ಸಂಖ್ಯೆ:ಉನಿಬಿ/ವಿ1/ಸಮಾಪನೆ/98-1999 ದಿನಾಂಕ: 26.11.1999.
2. ಸಹಕಾರ ಸಂಘಗಳ ಸಹಾಯಕ ನಿಬಂಧಕರು, ಬೀದರ್ ಉಪ ವಿಭಾಗ, ಬೀದರ್ ಇವರ ಪತ್ರ ಸಂಖ್ಯೆ/ಸನಿಬಿ1/ವಿ6/ ಸಮಾಪನೆ/ಸಿಆರ್ /2003-2004/ದಿನಾಂಕ 22.12.2003 ಹಾಗೂ 12.8.2005.

**ಪ್ರಸ್ತಾವನೆ:**

ಹಾಲು ಉತ್ಪಾದಕರ ಸಹಕಾರ ಸಂಘ ನಿ, ಹಾರಕೂಡ ತಾ।। ಬಸವಕಲ್ಯಾಣ ಈ ಸಂಘವು ಸಂಖ್ಯೆ/ಎಆರ್-1/ಎಸ್.4/ಜೆಓಟಿ/1831/ 93-94 ದಿನಾಂಕ:6.9.94ರಲ್ಲಿ ನೊಂದಣಿಯಾಗಿರುತ್ತದೆ. ಸಂಘದ ಕಾರ್ಯಚಟುವಟಿಕೆಗಳು ಪೂರ್ಣ ಸ್ಥಗಿತಗೊಂಡಿದ್ದರಿಂದ ಈ ಸಂಘವನ್ನು ಮುಂದುವರಿಸಿಕೊಂಡು ಹೋಗುವುದು ಸೂಕ್ತವಲ್ಲವೆಂದು ಭಾವಿಸಿ, ಉಲ್ಲೇಖ (1)ರ ಆದೇಶದಲ್ಲಿ ಸಮಾಪನೆಗೊಳಿಸಿ ಮಾರ್ಗ ವಿಸ್ತೀರ್ಣಾಧಿಕಾರಿ ಕೆ.ಎಂ.ಎಫ್. ಇವರನ್ನು ಸಮಾಪನಾಧಿಕಾರಿಯನ್ನಾಗಿ ನೇಮಕ ಮಾಡಲಾಗಿತ್ತು. ಸಮಾಪನಾಧಿಕಾರಿಗಳು ಸಂಘದ ನೊಂದಣಿ ಸಂಖ್ಯೆ ರದ್ದುಪಡಿಸಲು ಸಹಕಾರ ಸಂಘಗಳ ಸಹಾಯಕ ನಿಬಂಧಕರು, ಬೀದರ್ ಇವರ ಮೂಲಕ ಉಲ್ಲೇಖ (2)ರ ಮುಖೇನ ಪ್ರಸ್ತಾವನೆ ಸಲ್ಲಿಸಿರುತ್ತಾರೆ. ಸಹಕಾರ ಸಂಘಗಳ ಸಹಾಯಕ ನಿಬಂಧಕರು, ಬೀದರ್ ಇವರು ಸಂಘದಲ್ಲಿ ಯಾವುದೇ ಆಸ್ತಿ-ಜವಾಬ್ದಾರಿ ಇರುವುದಿಲ್ಲ ಮತ್ತು ಸಂಘದಿಂದ ಸರ್ಕಾರಕ್ಕೆ ಬರಬೇಕಾದ ಯಾವುದೇ ಬಾಕಿ ಇಲ್ಲವೆಂದು ಪ್ರಮಾಣ ಪತ್ರ ನೀಡಿರುತ್ತಾರೆ. ಹಾಗೂ ಸಂಘದ ಹೆಸರಿನಲ್ಲಿ ಇರುವ ಶಿಲ್ಕು ಹಣವನ್ನು ಉಪ ನಿಬಂಧಕರ ಪಿ.ಡಿ. ಖಾತೆಗೆ ವರ್ಗಾಯಿಸಿ ಸಂಘದ ನೊಂದಣಿ ಸಂಖ್ಯೆ ರದ್ದುಪಡಿಸಲು ಶಿಫಾರಸ್ಸು ಮಾಡಿರುತ್ತಾರೆ. ಈ ಅಂಶಗಳನ್ನು ಪರಿಗಣಿಸಿ ಕೆಳಕಂಡ ಆದೇಶ ಹೊರಡಿಸಲಾಗಿದೆ.

**ಆದೇಶ**

**ಸಂಖ್ಯೆ/ಉನಿಬಿ/ವಿ2/ಸಮಾಪನೆ/ಸಿಆರ್- /2005-2006/2228, ದಿನಾಂಕ: 30ನೇ ಆಗಸ್ಟ್ 2005**

ಪ್ರಸ್ತಾವನೆಯಲ್ಲಿನ ಅಂಶಗಳನ್ನು ಪರಿಗಣಿಸಿ, ಕರ್ನಾಟಕ ಸಹಕಾರ ಸಂಘಗಳ ಕಾಯ್ದೆ 1959ರ ಕಲಂ 75 ರನ್ವಯ ಹಾಗೂ ಸರ್ಕಾರಿ ಅಧಿಸೂಚನೆ ಸಂಖ್ಯೆ ಸಿಎಂಡಬ್ಲ್ಯೂ/69/ಸಿಎಲ್ಎಂ/200/ದಿನಾಂಕ:21.11.2001 ರಲ್ಲಿ ದತ್ತವಾಗಿರುವ ಅಧಿಕಾರವನ್ನು ಚಲಾಯಿಸುತ್ತಾ **ಎಂ.ಡಿ. ಮಠಪತಿ** ಸಹಕಾರ ಸಂಘಗಳ ಉಪ ನಿಬಂಧಕರು, ಬೀದರ್ ಜಿಲ್ಲೆ ಬೀದರ್ ಆದ ನಾನು ಸಮಾಪನೆಗೊಂಡ ಹಾಲು ಉತ್ಪಾದಕರ ಸಹಕಾರ ಸಂಘ ನಿ, ಹಾರಕೂಡ ತಾ।। ಬಸವಕಲ್ಯಾಣ ಇದರ ನೊಂದಣಿ ಸಂಖ್ಯೆ/ಎಆರ್-1/ಎಸ್.4/ಜೆಓಟಿ/1831/93-94 ದಿನಾಂಕ:6.9.94ನ್ನು ರದ್ದುಗೊಳಿಸಿ ಆದೇಶ ಹೊರಡಿಸಿರುತ್ತೇನೆ.

ಈ ರದ್ದತಿಯ ಆದೇಶದ ದಿನಾಂಕದಿಂದ ಸದರಿ ಸಹಕಾರ ಸಂಘದ ಕಾರ್ಯಾಚಟುವಟಿಕೆಗಳು ನಿಂತುಹೋಗಿರುತ್ತವೆಂದು ಭಾವಿಸತಕ್ಕದ್ದು. ಹಾಗೂ ಈ ಸಂಘವು ಅಸ್ತಿತ್ವದಲ್ಲಿರುವುದಿಲ್ಲವೆಂದು ಪರಿಗಣಿಸತಕ್ಕದ್ದು. ಹಾಗೂ ಕರ್ನಾಟಕ ಸಹಕಾರ ಸಂಘಗಳ ನಿಯಮಗಳ 1960ರ ನಿಯಮ 33 (ಎನ್) ರನ್ವಯ ಈ ಸಂಘದ ದಾಖಲಾತಿಗಳನ್ನು ಸಹಕಾರ ಸಂಘಗಳ ಸಹಾಯಕ ನಿಬಂಧಕರು, ಬೀದರ್ ಇವರ ಕಛೇರಿಯಲ್ಲಿಡಲು ಆದೇಶಿಸಿದೆ.

ನನ್ನ ಸ್ವ ಸಹಿ ಮತ್ತು ಈ ಕಛೇರಿ ಮುದ್ರೆಯೊಂದಿಗೆ ದಿನಾಂಕ: 20.8.2005 ರಂದು ಈ ಆದೇಶವನ್ನು ಹೊರಡಿಸಲಾಗಿದೆ.

ಪಿ.ಆರ್. 1270 ಸಹಕಾರ ಸಂಘಗಳ ಉಪ ನಿಬಂಧಕರು, ಬೀದರ್.

## ಜಿಲ್ಲಾಧಿಕಾರಿಗಳು ಬೆಂಗಳೂರು ಜಿಲ್ಲೆ, ಬೆಂಗಳೂರು

**ಅಂತಿಮ ಅಧಿಸೂಚನೆ ನಂ.ಕೆ.ಎಸ್.ಎ.:ಸಿ.ಆರ್:41/03-04, ದಿನಾಂಕ: 27ನೇ ಆಗಸ್ಟ್ 2005**

ನಂ.ಕೆ.ಎಸ್.ಎ:ಸಿ.ಆರ್:41/03-04, ದಿನಾಂಕ: 12.5.2004ರ ಪ್ರಿಲಿಮಿನರಿ ಅಧಿಸೂಚನೆಯನ್ನು ಕರ್ನಾಟಕ ರಾಜ್ಯಪತ್ರದಲ್ಲಿ ಪ್ರಕಟಿಸಿ ಅದರಲ್ಲಿ ಸದರಿ ಅಧಿಸೂಚನೆಯ ಷೆಡ್ಯೂಲ್‌ನಲ್ಲಿರುವ ಬೆಂಗಳೂರು ನಗರ ರಾಗಿಗುಡ್ಡ ಕೊಳಚೆ ಪ್ರದೇಶ, ನೈನಪ್ಪಶೆಟ್ಟಿಪಾಳ್ಯ, ಜೆ.ಪಿ. ನಗರ, ಬೆಂಗಳೂರುವನ್ನು ಕರ್ನಾಟಕ ಕೊಳಚೆ ಪ್ರದೇಶಗಳ (ನಿರ್ಮೂಲನೆ ಮತ್ತು ಅಭಿವೃದ್ಧಿ) ಕಾಯ್ದೆ 1973ರ ಸೆಕ್ಷನ್ 3 ರಡಿಯಲ್ಲಿ ಪ್ರಾರಂಭಿಕವಾಗಿ ಕೊಳಚೆ ಪ್ರದೇಶವೆಂದು ಘೋಷಿಸಿ ಸಂಬಂಧಿಸಿದವರಿಂದ ಆಕ್ಷೇಪಣೆಗಳನ್ನು ಆಹ್ವಾನಿಸಲಾಗಿತ್ತು.

ಸದರಿ ಪ್ರಿಲಿಮಿನರಿ ಅಧಿಸೂಚನೆಗೆ ಸಂಬಂಧಿಸಿದಂತೆ ಆಕ್ಷೇಪಣೆಗಳು ಯಾವುದೂ ಬಂದಿರುವುದಿಲ್ಲ. ಈ ಬಗ್ಗೆ ಆಯುಕ್ತರು, ಕರ್ನಾಟಕ ಕೊಳಚೆ ನಿರ್ಮೂಲನಾ ಮಂಡಳಿಯವರು ವರದಿ ಸಲ್ಲಿಸಿ ಈ ಪ್ರದೇಶದಲ್ಲಿ ಗುಡಿಸಲು ಇರುವುದರಿಂದ ಹಾಗೂ ಈ ಪ್ರದೇಶವು ಕೊಳಚೆ ಗುಣಲಕ್ಷಣಗಳನ್ನು ಹೊಂದಿರುವುದರಿಂದ ಇದನ್ನು ಕೊಳಚೆ ಪ್ರದೇಶವೆಂದು ಅಂತಿಮವಾಗಿ ಘೋಷಿಸುವಂತೆ ತಿಳಿಸಿರುತ್ತಾರೆ.

ಪ್ರಶ್ನಿತ ಕೊಳಚೆ ಪ್ರದೇಶದಲ್ಲಿ ಗುಡಿಸಲು/ಮನೆಗಳು ದುರಸ್ಥಿ ಇಲ್ಲದೇ ಕುಡಿಯುವ ನೀರು, ದೀಪ, ರಸ್ತೆ, ಚರಂಡಿ ಇತ್ಯಾದಿ ಮೂಲಭೂತ ಸೌಕರ್ಯಗಳಿಲ್ಲದೇ ಅನಾರೋಗ್ಯದ ವಾತಾವರಣ ಉಂಟಾಗಿರುತ್ತದೆ. ಸದರಿ ಪ್ರದೇಶವನ್ನು ಅಭಿವೃದ್ಧಿಪಡಿಸುವುದು ಅತ್ಯಗತ್ಯವಾಗಿರುತ್ತದೆ. ಆದ್ದರಿಂದ

ಕರ್ನಾಟಕ ಕೊಳಚೆ ಪ್ರದೇಶಗಳ (ಅಭಿವೃದ್ಧಿ ಮತ್ತು ನಿರ್ಮೂಲನೆ) ಕಾಯ್ದೆ 1973ರ ಸೆಕ್ಷನ್ 3 ರಡಿಯಲ್ಲಿ ದತ್ತವಾಗಿರುವ ಅಧಿಕಾರದಂತೆ ಈ ಕೆಳಕಂಡ ಷೆಡ್ಯೂಲ್‌ನಲ್ಲಿ ನಮೂದಿಸಿರುವ ಪ್ರದೇಶವನ್ನು ಮೇಲ್ಕಂಡ ಕಾಯ್ದೆಯ ಸೆಕ್ಷನ್ 3 ರಡಿಯಲ್ಲಿ ಅಂತಿಮವಾಗಿ ಕೊಳಚೆ ಪ್ರದೇಶವೆಂದು ಘೋಷಿಸಿರುತ್ತೇನೆ.

**ಷೆಡ್ಯೂಲ್**

ಬೆಂಗಳೂರು ನಗರ ಕಾರ್ಪೋರೇಷನ್ ವ್ಯಾಪ್ತಿಯ ಜೆ.ಪಿ. ನಗರ ಬಳಿಯಿರುವ ನೈನಪ್ಪಶೆಟ್ಟಿ ಪಾಳ್ಯದ ರಾಗಿಗುಡ್ಡ ಕೊಳಚೆ ಪ್ರದೇಶದ ವಿವರ ಮತ್ತು ಚೆಕ್ಕುಬಂದಿ ತಃಖ್ತೆ.

| ಕ್ರ. ಸಂ. | ಕೊಳಚೆ ಪ್ರದೇಶದ ಹೆಸರು ಮತ್ತು ಸ್ಥಳ | ಮಾಲೀಕರ ಹೆಸರು | ಸರ್ವೆ ನಂ. | ವಿಸ್ತೀರ್ಣ (ಎ.ಗುಂ) | ಚೆಕ್ಕುಬಂದಿಗಳು | | | |
|---|---|---|---|---|---|---|---|---|
| | | | | | ಪೂರ್ವ | ಪಶ್ಚಿಮ | ಉತ್ತರ | ದಕ್ಷಿಣ |
| 1 | ರಾಗಿಗುಡ್ಡ ಕೊಳಚೆ ಪ್ರದೇಶ, ನೈನಪ್ಪಶೆಟ್ಟಿಪಾಳ್ಯ, ಜೆ.ಪಿ.ನಗರ, ಬೆಂಗಳೂರು | 1) ಕೆ.ಎಸ್.ಆರ್.ಟಿ.ಸಿ. ಸೆಂಟ್ರಲ್ ಆಫೀಸ್ ಹೌಸಿಂಗ್ ಕೋ ಆಪರೇಟಿವ್ ಸೊಸೈಟಿ ಮತ್ತು ಬಿ.ಡಿ.ಎ. | 93 | 1.08 | ರಸ್ತೆ ಮತ್ತು ಕೆ.ಎಸ್.ಆರ್.ಟಿ.ಸಿ. ಬಡಾವಣೆ | ರಸ್ತೆ ಮತ್ತು ಕೆ.ಎಸ್.ಆರ್.ಟಿ.ಸಿ. ಬಡಾವಣೆ | ರಸ್ತೆ | 8ನೇ ಮುಖ್ಯ ರಸ್ತೆ |
| | | 2) ವಿ. ನಾರಾಯಣಸ್ವಾಮಿ ಮತ್ತು ಬಿ.ಡಿ.ಎ. | 94 | 0.37 | | | | |
| | | 3) ಎ. ಜಯಮ್ಮ ಮತ್ತು ಬಿ.ಡಿ.ಎ. | 95 | 1.12 | | | | |
| | | 4) ಖಾತೆದಾರರ ಹೆಸರು ನಮೂದಿಸಿಲ್ಲ ಮತ್ತು ಬಿ.ಡಿ.ಎ. | 98/1,2 | 3.02 | | | | |

**ಎಂ.ಎ. ಸಾಧಿಕ್**

ಜಿಲ್ಲಾಧಿಕಾರಿಗಳು, ಬೆಂಗಳೂರು ಜಿಲ್ಲೆ, ಬೆಂಗಳೂರು.

ಪಿ.ಆರ್. 1271

## ಆಹಾರ, ನಾಗರೀಕ ಸರಬರಾಜು ಮತ್ತು ಗ್ರಾಹಕರ ವ್ಯವಹಾರಗಳ ಇಲಾಖೆ

**ಅಧಿಸೂಚನೆ ಸಂಖ್ಯೆ: ಆನಾಸ 141 ಸಲಫ 2004, ದಿನಾಂಕ: 20ನೇ ಆಗಸ್ಟ್ 2005**

ಗ್ರಾಹಕರ ರಕ್ಷಣಾ ಅಧಿನಿಯಮ 1986 (1986 ಕೇಂದ್ರ ಅಧಿನಿಯಮ ಸಂಖ್ಯೆ: 68)ರ ಕಲಂ 30ರ ಉಪ ಕಲಂ (2)ರ ಅಡಿ; ಮತ್ತು ಕರ್ನಾಟಕ ಗ್ರಾಹಕರ ರಕ್ಷಣಾ ನಿಯಮಾವಳಿಗಳು, 1988ರ ನಿಯಮ 2ಸಿ ಅಡಿ ಪ್ರದತ್ತವಾಗಿರುವ ಅಧಿಕಾರಗಳನ್ನು ಚಲಾಯಿಸಿ; "ಬಳ್ಳಾರಿ ಜಿಲ್ಲಾ ಗ್ರಾಹಕರ ರಕ್ಷಣಾ ಪರಿಷತ್ತು" ಎಂಬ ಪರಿಷತ್ತನ್ನು ಈ ಕೆಳಕಂಡ ಸದಸ್ಯರುಗಳೊಂದಿಗೆ ಈ ಮೂಲಕ ಸ್ಥಾಪಿಸುತ್ತಿದೆ:-

| | | |
|---|---|---|
| 1) | ಜಿಲ್ಲಾಧಿಕಾರಿಗಳು, ಬಳ್ಳಾರಿ ಜಿಲ್ಲೆ, ಬಳ್ಳಾರಿ. | ಅಧ್ಯಕ್ಷರು |
| 2) | ಉಪ ನಿರ್ದೇಶಕರು, ಆಹಾರ, ನಾಗರೀಕ ಸರಬರಾಜು ಮತ್ತು ಗ್ರಾಹಕರ ವ್ಯವಹಾರಗಳ ಇಲಾಖೆ, ಬಳ್ಳಾರಿ ಜಿಲ್ಲೆ. | ಸದಸ್ಯ ಕಾರ್ಯದರ್ಶಿ |
| | **ಸಕ್ರಿಯ ಗ್ರಾಹಕ ಸಂಸ್ಥೆಗಳು:** | |
| 3) | ಕಾರ್ಯದರ್ಶಿ, ಬಳ್ಳಾರಿ ನಾಗರೀಕ ವೇದಿಕೆ, ಕಪ್ಪಗಲ್ ರಸ್ತೆ, ಬಳ್ಳಾರಿ. | ಸದಸ್ಯರು |
| 4) | ಅಧ್ಯಕ್ಷರು, ನಾಗರೀಕ ಬಳಕೆದಾರರ ವೇದಿಕೆ, ಉಜ್ಜಿನಿ ರೋಡ್, 6ನೇ ವಾರ್ಡು, ಕೋಳ್ಳಿಪಂಪಣ ಓಣಿ, ಕೊಟ್ಟೂರು, ಕೂಡ್ಲಿಗಿ ತಾಲ್ಲೂಕು. | ಸದಸ್ಯರು |
| | **ಮಹಿಳಾ ಸಹಕಾರಿ ಸಂಘ:** | |
| 5) | ಶ್ರೀಮತಿ ಮಹಬುನ್ನಿಸಾ, ಅಧ್ಯಕ್ಷರು, ಮಹಿಳಾ ವಿವಿಧೋದ್ದೇಶ ಸಹಕಾರಿ ಸಂಘ ನಿಯಮಿತ, ಜಂಡಕಟ್ಟ, 25ನೇ ವಾರ್ಡು, ಕಾರ್ಖಿಸಕುಂಟ, ಬಳ್ಳಾರಿ. | ಸದಸ್ಯರು |
| | **ರೈತ ಸಂಘ ಸಂಸ್ಥೆ:** | |
| 6) | ಅಧ್ಯಕ್ಷರು, ಹೊಸಪೇಟೆ ರೈತರ ಸಂಘ (ರಿ), ರಿ.ನಂ.34/75-76, ಐಎಸ್‌ಆರ್ ರಸ್ತೆ, ಚಿತವಾಡಿಗಿ, ಹೊಸಪೇಟೆ. | ಸದಸ್ಯರು |
| 7) | ಕಾರ್ಯದರ್ಶಿ, ತಾಲ್ಲೂಕು ಕೃಷಿಕ ಸಮಾಜ, (ಸ.ನಿ.ಕಛೇರಿ), ತಾಲ್ಲೂಕು ಕಛೇರಿ ಆವರಣ, ಬಳ್ಳಾರಿ. | ಸದಸ್ಯರು |
| | **ವಾಣಿಜ್ಯ ವ್ಯಾಪಾರ:** | |
| 8) | ಶ್ರೀ ಡಿ.ಎಸ್. ಜ್ಞಾನಮೂರ್ತಿ, ಶಾಂತಿಧಾಮ, ತಾಳೂರು ರಸ್ತೆ, ಪಾರ್ವತಿನಗರ, ಬಳ್ಳಾರಿ. | ಸದಸ್ಯರು |
| | **ಸ್ತ್ರೀಶಕ್ತಿ ಸಂಸ್ಥೆಯ ಅಧ್ಯಕ್ಷರು:** | |
| 9) | ಶ್ರೀಮತಿ ಮಂಗಳಗೌರಮ್ಮ ಅನ್ನಪೂರ್ಣೇಶ್ವರಿ ಸ್ತ್ರೀಶಕ್ತಿ, ಗುಂಪು, ತಾರಾನಗರ, ಸಂಡೂರು ತಾಲ್ಲೂಕು. | ಸದಸ್ಯರು |
| | **ಯುವಜನ ಸಂಘ ಸಂಸ್ಥೆಗಳು:** | |
| 10) | ಶ್ರೀ ಜಂಬನಗೌಡ ಬಸವೇಶ್ವರ ಯುವಕ ಸಂಘ, ಶ್ರೀಧರ ಗಡ್ಡ, ಬಳ್ಳಾರಿ ತಾಲ್ಲೂಕು. | ಸದಸ್ಯರು |
| | **ಸರ್ಕಾರದ ನಾಮ ನಿರ್ದೇಶಿತ ಸದಸ್ಯರು** | |
| 11) | ಶ್ರೀ ಮುದೇಗೌಡ್ರ ಚಂದ್ರಪ್ಪ ತಂದೆ ಬಸಪ್ಪ, ಅಂಬಳಿ, ಹಗರಿಬೊಮ್ಮನಹಳ್ಳಿ, ಬಳ್ಳಾರಿ ಜಿಲ್ಲೆ. | ಸದಸ್ಯರು |
| 12) | ಶ್ರೀ ಹನುಮಂತಪ್ಪ, ಪ್ರಧಾನ ಕಾರ್ಯದರ್ಶಿ, ಜಿಲ್ಲಾ ಜನತಾ ದಳ (ಜಾತ್ಯಾತೀತ) ಕಾರ್ಯಾಲಯ, ಬಳ್ಳಾರಿ. | ಸದಸ್ಯರು |

2) ಈ ಅಧಿಸೂಚನೆ ಕರ್ನಾಟಕ ರಾಜ್ಯ ಪತ್ರದಲ್ಲಿ ಪ್ರಕಟವಾದ ದಿನಾಂಕದಿಂದ ಮೂರು ವರ್ಷಗಳ ಅವಧಿಗೆ ಅಥವಾ ಸರ್ಕಾರದ ಮುಂದಿನ ಆದೇಶದವರೆಗೆ, ಇವೆರಡರಲ್ಲಿ ಯಾವುದು ಮೊದಲೋ ಅಲ್ಲಿಯವರೆಗೆ, ಈ ಜಿಲ್ಲಾ ಗ್ರಾಹಕರ ಪರಿಷತ್ತು ತನ್ನ ಕಾರ್ಯಾವಧಿಯನ್ನು ಹೊಂದಿರುತ್ತದೆ.

3) ಈ ಪರಿಷತ್ತು ಕರ್ನಾಟಕ ಗ್ರಾಹಕರ ರಕ್ಷಣಾ ನಿಯಮಾವಳಿಗಳು 1988ರ ನಿಯಮ 2ಡಿ ಅಡಿ ವಿಧಿಸಿರುವ ವಿಧಾನದಂತೆ ಕಾರ್ಯ ನಿರ್ವಹಿಸತಕ್ಕದ್ದು.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 1214

ಎ.ಎಸ್. ವಿಶ್ವೇಶ್ವರಯ್ಯ

ಪೀಠಾಧಿಕಾರಿ (ಪ್ರಭಾರ), ಆಹಾರ-3 ಶಾಖೆ,

ಆಹಾರ, ನಾಗರೀಕ ಸರಬರಾಜು ಮತ್ತು ಗ್ರಾಹಕರ ವ್ಯವಹಾರಗಳ ಇಲಾಖೆ.

## ಭಾಷಾಂತರ ನಿರ್ದೇಶನಾಲಯ

### 3ನೇ ಮಹಡಿ, 'ಎಫ್' ಬ್ಲಾಕ್, ಸಿಬಿಎಬಿ ಕಾಂಪ್ಲೆಕ್ಸ್, ಕಾವೇರಿ ಭವನ, ಕೆ.ಜಿ. ರಸ್ತೆ, ಬೆಂಗಳೂರು-9

### ಅಧಿಸೂಚನೆ ಸಂಖ್ಯೆ: ಭಾನಿ:63:ಆಡಳಿತ:ಮಾಹಅ:2005, ದಿನಾಂಕ: 11ನೇ ಆಗಸ್ಟ್ 2005

ಮಾಹಿತಿ ಪಡೆಯಲು ಹಕ್ಕು ಅಧಿನಿಯಮ, 2005 (ಕೇಂದ್ರ ಅಧಿನಿಯಮ ಸಂಖ್ಯೆ 2005ರ 22) ಪ್ರಕರಣ 2 ಖಂಡ (ಹೆಚ್) ಉಪಖಂಡ (ಸಿ) ಮತ್ತು (ಡಿ) ಮೇರೆಗೆ ಹಾಗೂ ಪ್ರಕರಣ 5ರ (1) ಮತ್ತು (2)ನೇ ಖಂಡದ ಮೇರೆಗೆ ಭಾಷಾಂತರ ನಿರ್ದೇಶನಾಲಯಕ್ಕೆ ಸಂಬಂಧಿಸಿದಂತೆ ಈ ಕೆಳಕಂಡಂತೆ ಪ್ರಾಧಿಕಾರವನ್ನು ಮತ್ತು ಪ್ರಾಧಿಕಾರಿಗಳನ್ನು ತಕ್ಷಣದಿಂದ ಜಾರಿಗೆ ಬರುವಂತೆ ಗೊತ್ತುಪಡಿಸಲಾಗಿದೆ.

| | |
|---|---|
| ಭಾಷಾಂತರ ನಿರ್ದೇಶನಾಲಯ,<br>3ನೇ ಮಹಡಿ 'ಎಫ್' ಬ್ಲಾಕ್, ಸಿಬಿಎಬಿ ಕಾಂಪ್ಲೆಕ್ಸ್,<br>ಕಾವೇರಿಭವನ, ಕೆ.ಜಿ. ರಸ್ತೆ, ಬೆಂಗಳೂರು-9 | ಸಾರ್ವಜನಿಕ ಪ್ರಾಧಿಕಾರ |
| ಸಹಾಯಕ ಆಡಳಿತಾಧಿಕಾರಿ,<br>ಭಾಷಾಂತರ ನಿರ್ದೇಶನಾಲಯ,<br>ಬೆಂಗಳೂರು. | ರಾಜ್ಯ ಸಹಾಯಕ ಸಾರ್ವಜನಿಕ<br>ಮಾಹಿತಿ ಅಧಿಕಾರಿ |
| ಉಪ ನಿರ್ದೇಶಕರು (ಆಡಳಿತ)<br>ಭಾಷಾಂತರ ನಿರ್ದೇಶನಾಲಯ, ಬೆಂಗಳೂರು. | ರಾಜ್ಯ ಸಾರ್ವಜನಿಕ ಮಾಹಿತಿ ಅಧಿಕಾರಿ |
| ನಿರ್ದೇಶಕರು,<br>ಭಾಷಾಂತರ ನಿರ್ದೇಶನಾಲಯ, ಬೆಂಗಳೂರು. | ಮೊದಲ ಅಪೀಲು ಅಧಿಕಾರಿ |

ಪಿ.ಆರ್. 1274

ನಿರ್ದೇಶಕರು.

## ಕಂದಾಯ ಇಲಾಖೆ

### ಅಧಿಸೂಚನೆ ಸಂಖ್ಯೆ: ಕಂಇ 59 ಆರ್‌ಇಹೆಚ್ 04, ಬೆಂಗಳೂರು, ದಿನಾಂಕ: 20ನೇ ಆಗಸ್ಟ್ 2005

ತುಂಗಾ ಮೇಲ್ದಂಡೆ ಯೋಜನೆಯಿಂದ ಮುಳುಗಡೆಯಾಗಲಿರುವ ನಿರಾಶ್ರಿರಾದ ಜನರಿಗೆ ಪುನರ್ವಸತಿ:ಪುನರ್ ನಿರ್ಮಾಣ ಕಲ್ಪಿಸಲು ಸೂಕ್ತ ಪುನರ್ವಸತಿ:ಪುನರ್ ನಿರ್ಮಾಣ ಪರಿಹಾರಗಳ ಬಗ್ಗೆ ಶಿಫಾರಸ್ಸು ಮಾಡಲು ದಿನಾಂಕ:18.10.01 ರಂದು ಹೊರಡಿಸಲಾದ ಅಧಿಸೂಚನೆಯನ್ನು ಪರಿಷ್ಕರಿಸಿ ಈ ಕೆಳಕಂಡ ಅಧಿಕಾರಿ ಮತ್ತು ಅಧಿಕಾರೇತರ ಸದಸ್ಯರನ್ನೊಳಗೊಂಡ ತುಂಗಾ ಮೇಲ್ದಂಡೆ ಯೋಜನೆ ಪುನರ್ವಸತಿ ಸಲಹಾ ಸಮಿತಿಯನ್ನು ಪುನರ್ ರಚಿಸಿ, ಈ ಆದೇಶ ಹೊರಡಿಸಲಾಗಿದೆ.

**ಅಧಿಕಾರೇತರರು**

| | | |
|---|---|---|
| 1) | ಜಿಲ್ಲಾ ಉಸ್ತುವಾರಿ ಸಚಿವರು | ಅಧ್ಯಕ್ಷರು |
| 2) | ಶ್ರೀ ಎಸ್. ಬಂಗಾರಪ್ಪ, ಲೋಕ ಸಭಾಸದಸ್ಯರು, ಶಿವಮೊಗ್ಗ ಕ್ಷೇತ್ರ | ಸದಸ್ಯರು |
| 3) | ಶ್ರೀ ಬಿ.ಎಸ್. ಯಡಿಯೂರಪ್ಪ, ವಿಧಾನ ಸಭಾ ಸದಸ್ಯರು, ಶಿಕಾರಿಪುರ | ಸದಸ್ಯರು |
| 4) | ಶ್ರೀ ಪಿ.ಕೆ. ಸಂಗಮೇಶ್ವರ, ವಿಧಾನ ಸಭಾ ಸದಸ್ಯರು, ಭದ್ರಾವತಿ | ಸದಸ್ಯರು |
| 5) | ಶ್ರೀ ಬಸವಣ್ಣಪ್ಪ .ಜಿ, ವಿಧಾನ ಸಭಾ ಸದಸ್ಯರು, ಹೊಳೆಹೊನ್ನೂರು | ಸದಸ್ಯರು |
| 6) | ಶ್ರೀ ಕೆ.ಎಸ್. ಈಶ್ವರಪ್ಪ, ವಿಧಾನ ಸಭಾ ಸದಸ್ಯರು, ಶಿವಮೊಗ್ಗ | ಸದಸ್ಯರು |
| 7) | ಶ್ರೀ ಅರಗ ಜ್ಞಾನೇಂದ್ರ, ವಿಧಾನ ಸಭಾ ಸದಸ್ಯರು, ತೀರ್ಥಹಳ್ಳಿ | ಸದಸ್ಯರು |
| 8) | ಶ್ರೀ ಹೆಚ್. ಹಾಲಪ್ಪ, ವಿಧಾನ ಸಭಾ ಸದಸ್ಯರು, ಹೊಸನಗರ | ಸದಸ್ಯರು |
| 9) | ಶ್ರೀ ಬಿ.ಕೆ. ಗೋಪಾಲಕೃಷ್ಣ ಬೇಳೂರು, ವಿಧಾನ ಸಭಾ ಸದಸ್ಯರು, ಸಾಗರ | ಸದಸ್ಯರು |
| 10) | ಶ್ರೀ ಕುಮಾರ ಬಂಗಾರಪ್ಪ, ವಿಧಾನ ಸಭಾ ಸದಸ್ಯರು, ಸೊರಬ | ಸದಸ್ಯರು |
| 11) | ಶ್ರೀ ಡಿ.ಹೆಚ್. ಶಂಕರಮೂರ್ತಿ, ವಿಧಾನ ಪರಿಷತ್ ಸದಸ್ಯರು | ಸದಸ್ಯರು |
| 12) | ಶ್ರೀ ಅಜೀಜ್ ಅಹ್ಮದ್, ವಿಧಾನ ಪರಿಷತ್ ಸದಸ್ಯರು | ಸದಸ್ಯರು |
| 13) | ಶ್ರೀ ಹೆಚ್.ಜಿ. ಬಾಲಕೃಷ್ಣಭಟ್ಟ, ವಿಧಾನ ಪರಿಷತ್ ಸದಸ್ಯರು | ಸದಸ್ಯರು |

**ಅಧಿಕಾರಿ ಸದಸ್ಯರು**

| | | |
|---|---|---|
| 1) | ಜಿಲ್ಲಾಧಿಕಾರಿಗಳು, ಶಿವಮೊಗ್ಗ ಜಿಲ್ಲೆ | ಸದಸ್ಯ ಕಾರ್ಯದರ್ಶಿ |
| 2) | ಮುಖ್ಯ ಇಂಜಿನಿಯರ್, ತುಂಗಾಮೇಲ್ದಂಡೆ ಯೋಜನೆ | ಸದಸ್ಯರು |
| 3) | ಜಿಲ್ಲಾ ಅರಣ್ಯ ಅಧಿಕಾರಿಗಳು, ಶಿವಮೊಗ್ಗ | ಸದಸ್ಯರು |
| 4) | ಕಾರ್ಯನಿರ್ವಾಹಕ ಅಭಿಯಂತರರು, ಲೋಕೋಪಯೋಗಿ ಇಲಾಖೆ | ಸದಸ್ಯರು |
| 5) | ಕಾರ್ಯನಿರ್ವಾಹಕ ಅಭಿಯಂತರರು, ಕರ್ನಾಟಕ ವಿದ್ಯುತ್ ಸರಬರಾಜು ನಿಗಮ ನಿಯಮಿತ. | ಸದಸ್ಯರು |

6) ಉಪ ವಿಭಾಗಾಧಿಕಾರಿಗಳು, ಶಿವಮೊಗ್ಗ ಸದಸ್ಯರು
7) ಉಪ ನಿರ್ದೇಶಕರು, ಕೃಷಿ ಇಲಾಖೆ ಸದಸ್ಯರು
8) ವಿಶೇಷ ಭೂ ಸ್ವಾಧೀನಾಧಿಕಾರಿಗಳು, ತುಂಗಾಮೇಲ್ದಂಡೆ ಯೋಜನೆ, ಶಿವಮೊಗ್ಗ ಸದಸ್ಯರು
9) ತಹಶೀಲ್ದಾರ್, ತೀರ್ಥಹಳ್ಳಿ ಸದಸ್ಯರು

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 1275

**ಎಸ್.ಎಂ. ಪಟ್ಟಣಶೆಟ್ಟಿ**

ಸರ್ಕಾರದ ಅಧೀನ ಕಾರ್ಯದರ್ಶಿ, (ಪ್ರಭಾರ) ಕಂದಾಯ ಇಲಾಖೆ. (ಪುನರ್ವಸತಿ)

## ಅಭಿಯೋಗ ಮತ್ತು ಸರ್ಕಾರಿ ವ್ಯಾಜ್ಯಗಳ ನಿರ್ದೇಶಕರ ಕಛೇರಿಯ ನಡವಳಿಗಳು ಬೆಂಗಳೂರು

**ವಿಷಯ:** ಶ್ರೀ ಕೆ.ಎಸ್. ರವೀಂದ್ರಗೌಡ, ಸಹಾಯಕ ಸರ್ಕಾರಿ ಅಭಿಯೋಜಕರು, 3ನೇ ಅಧಿಕ ಸಿ.ಜೆ.ಎಂ. ನ್ಯಾಯಾಲಯ, ಮೈಸೂರು, ಇವರನ್ನು ವಿಚಾರಣೆ ಬಾಕಿ ಇರಿಸಿ ಸೇವೆಯಿಂದ ಅಮಾನತ್ತಿನಲ್ಲಿಡುವ ಕುರಿತು.

**ಉಲ್ಲೇಖ:** ಅಭಿಯೋಗ ಉಪನಿರ್ದೇಶಕರು, ಮೈಸೂರು ವಿಭಾಗ, ಮೈಸೂರು, ಅವರ ಪತ್ರ ಸಂಖ್ಯೆ:ಅಉನಿ:ಸಿಶಾ:64:2005-06, ದಿನಾಂಕ: 12ನೇ ಆಗಸ್ಟ್ 2005.

**ಪ್ರಸ್ತಾವನೆ:**

ಅಭಿಯೋಗ ಉಪನಿರ್ದೇಶಕರು, ಮೈಸೂರು ವಿಭಾಗ, ಮೈಸೂರು, ಇವರು ಉಲ್ಲೇಖಿತ ಪತ್ರದಲ್ಲಿ, ಶ್ರೀ ಕೆ.ಎಸ್. ರವೀಂದ್ರಗೌಡ, ಸಹಾಯಕ ಸರ್ಕಾರಿ ಅಭಿಯೋಜಕರು, ಮೈಸೂರು, ಅವರು ದಿನಾಂಕ: 10.8.2005 ರಂದು ರಾತ್ರಿ 7.00 ಘಂಟೆ ಸಮಯದಲ್ಲಿ ಮೈಸೂರಿನ ಹೋಟೆಲ್ ಮಯೂರ್ ಯಾತ್ರಿ ನಿವಾಸ್, ರೂಂ ನಂ. 4 ರಲ್ಲಿ ಫಿರ್ಯಾದಿ ಶ್ರೀ ಬಷೀರ್ ಅಹಮ್ಮದ್‌ಖಾನ್ ಅವರಿಂದ ರೂ. 5,000-00 (ರೂಪಾಯಿಗಳು ಐದು ಸಾವಿರ ಮಾತ್ರ) ಲಂಚವನ್ನು ಪಡೆಯುತ್ತಿದ್ದಾಗ ಲೋಕಾಯುಕ್ತ ಪೋಲೀಸರ ಬಲೆಗೆ ಸಿಕ್ಕು ಬಿದ್ದು, ಅವರ ಮೇಲೆ ಲೋಕಾಯುಕ್ತ ಪೋಲೀಸರು, ಮೈಸೂರು ವಿಭಾಗ, ಮೈಸೂರು, ಇವರು ಗುನ್ಹೆ ನಂ. 5:2005, ಕಲಂ 7, 13 (1)(ಡಿ) ಸಹ ಕಲಂ 13(2) ಲಂಚ ನಿರೋಧ ಕಾಯ್ದೆ 1988ರ ಮೇರೆಗೆ ಪ್ರಕರಣವನ್ನು ದಾಖಲು ಮಾಡಿಕೊಂಡಿರುವುದಾಗಿ ಹಾಗೂ ಸದರಿ ಅಧಿಕಾರಿಯನ್ನು ಬಂಧಿಸಿ, ಜಾಮೀನಿನ ಮೇಲೆ ಬಿಡುಗಡೆ ಮಾಡಲಾಗಿರುವ ಬಗ್ಗೆ ವರದಿಯನ್ನು ಸಲ್ಲಿಸಿರುತ್ತಾರೆ. ಸದರಿ ವರದಿಯನ್ವಯ ಹಾಗೂ ಫಿರ್ಯಾದುದಾರರು ನೀಡಿರುವ ದೂರಿನನ್ವಯ, ಸದರಿ ಅಧಿಕಾರಿಯವರು ಸಹಾಯಕ ಸರ್ಕಾರಿ ಅಭಿಯೋಜಕರ ಹುದ್ದೆಯಲ್ಲಿ ಮುಂದುವರೆಯುವುದು ಸಮಂಜಸವಾಗಿರುವುದಿಲ್ಲ. ಆದ್ದರಿಂದ, ಸದರಿ ಅಧಿಕಾರಿಯವರ ವಿರುದ್ಧ ಇಲಾಖಾ ವಿಚಾರಣೆ ಬಾಕಿ ಇರಿಸಿ, ಅವರನ್ನು ಅಮಾನತ್ತಿನಲ್ಲಿಡುವುದು ಅಪೇಕ್ಷಣೀಯವೆಂದು ಕಂಡುಬಂದಿರುವುದರಿಂದ, ಈ ಕೆಳಕಂಡಂತೆ ಆದೇಶ ಹೊರಡಿಸಲಾಗಿದೆ.

**ಆದೇಶ ಸಂಖ್ಯೆ: ಡಿಪಿಎನ್:ಸಿಶಾ-1:133:2005-2006, ಬೆಂಗಳೂರು, ದಿನಾಂಕ: 18ನೇ ಆಗಸ್ಟ್ 2005**

ಪ್ರಸ್ತಾವನೆಯಲ್ಲಿನ ಅಂಶಗಳನ್ನು ಕೂಲಂಕಷವಾಗಿ ಪರಿಶೀಲಿಸಿ, ಶ್ರೀ ಕೆ.ಎಸ್. ರವೀಂದ್ರಗೌಡ, ಸಹಾಯಕ ಸರ್ಕಾರಿ ಅಭಿಯೋಜಕರು, 3ನೇ ಅಧಿಕ ಸಿ.ಜೆ.ಎಂ. ನ್ಯಾಯಾಲಯ, ಮೈಸೂರು, ಇವರನ್ನು ಕರ್ನಾಟಕ ಸಿವಿಲ್ ಸೇವಾ (ವರ್ಗೀಕರಣ, ನಿಯಂತ್ರಣ ಮತ್ತು ಅಪೀಲು) ನಿಯಮಗಳು 1957ರ 10ನೇ ನಿಯಮದ (1) (ಎ) ಉಪ ನಿಯಮದಡಿ ಪ್ರದತ್ತವಾದ ಅಧಿಕಾರದನ್ವಯ, ಇವರ ವಿರುದ್ಧ ಇಲಾಖಾ ವಿಚಾರಣೆ ಬಾಕಿ ಇರಿಸಿ, ಈ ಕೂಡಲೇ ಜಾರಿಗೆ ಬರುವಂತೆ ಮತ್ತು ಮುಂದಿನ ಆದೇಶದವರೆಗೆ ಸೇವೆಯಿಂದ ಅಮಾನತ್ತಿನಲ್ಲಿಡಲಾಗಿದೆ.

ಅಮಾನತ್ತಿನ ಅವಧಿಯಲ್ಲಿ ಇವರು ನಿಯಮಾನುಸಾರ ಜೀವನಾಧಾರ ಭತ್ಯೆ ಪಡೆಯಲು ಅರ್ಹರಿರುತ್ತಾರೆ.

ಅಮಾನತ್ತಿನ ಅವಧಿಯಲ್ಲಿ ಶ್ರೀ ಕೆ.ಎಸ್. ರವೀಂದ್ರಗೌಡ, ಇವರು ಸಕ್ಷಮ ಪ್ರಾಧಿಕಾರದ ಅನುಮತಿ ಇಲ್ಲದೆ ತಮ್ಮ ಕೇಂದ್ರ ಸ್ಥಾನವನ್ನು ಬಿಡತಕ್ಕದ್ದಲ್ಲ.

**ಆರ್.ಜಿ. ದೇಸಾಯಿ**

ಪಿ.ಆರ್. 1276

ಅಭಿಯೋಗ ಮತ್ತು ಸರ್ಕಾರಿ ವ್ಯಾಜ್ಯಗಳ ನಿರ್ದೇಶಕರು, ಬೆಂಗಳೂರು.

## KARNATAKA POWER TRANSMISSION CORPORATION LIMITED

**Office of the Executive Engineer Elecl., Major Works Division, KPTCL., N.R. Mohalla, Mysore-7**

**DRAFT NOTIFICATION No: EEE/AEE (O)/MWD/MYS/2005-06, Dated: 4th August 2005**

Karnataka Power Transmission Corporation Limited has formulated a scheme under section 28 and clause (e) of section 18 of the Electricity supply Act 1948 and the scheme is herewith published in pursuance of section 29(2) of the said Act, this notification is issued for information of the license holders and any other concerned persons. Particulars of the scheme are as hereunder:

| | | |
|---|---|---|
| Name of the Work | : | Construction of Proposed 66KV line from the tapping point of existing Hunsur - Ponnampet 66KV SC line to the Proposed 66/11KV S/S at Hanagodu in Hunsur Taluk, Mysore District. |
| Salient Features and | : | To Improve Voltage condition & To meet future Load growth of Hanagodu & its Surrounding areas. |
| Areas Passing through | : | Hanagodu, Kamegoudanahalli & Hammige Limits. |
| Approximate length of the line | : | 3.202 Km. |
| Approximate Cost | : | 61.50 Lakhs. |

KPTCL shall have and exercise all powers which the telegraph authorities posses under part - III of the Indian Telegraph Act 1985 (13 of 1985) for implementation of the above said scheme. Any objections regarding the above scheme shall be sent to the Executive Engineer Elecl., Major works Division, KPTCL, Mysore-7 within two months from the date of Publication of this notification for KPTCL's, pursuance.

P.D. 76

Executive Engineer Elecl., KPTCL, M.W. Division, Mysore.

**ಕರ್ನಾಟಕ ರಾಜ್ಯ ಗ್ರಾಹಕರ ವ್ಯಾಜ್ಯಗಳ ಪರಿಹಾರ ಆಯೋಗ ಬಸವ ಭವನ, ಹೈಗ್ರೌಂಡ್ಸ್, ಬೆಂಗಳೂರು-1**

**ವಿಷಯ:** 2005ರ ಮಾಹಿತಿ ಹಕ್ಕು ಕಾಯ್ದೆ (2005ರ ಕೇಂದ್ರ ಕಾಯ್ದೆ ಸಂಖ್ಯೆ 22) ಯಡಿಯಲ್ಲಿ ಸಾರ್ವಜನಿಕ ಮಾಹಿತಿ ಅಧಿಕಾರಿ, ಸಹಾಯಕ ಸಾರ್ವಜನಿಕ ಮಾಹಿತಿ ಅಧಿಕಾರಿ ಹಾಗೂ ಮೇಲ್ಮನವಿ ಪ್ರಾಧಿಕಾರದ ನೇಮಕ ಕುರಿತು.

**ಓದಲಾಗಿದೆ:** ಸರ್ಕಾರದ ಪತ್ರ ಸಂಖ್ಯೆ ಅನಾಸ:119:ಇಭತ:2005, ದಿನಾಂಕ: 20.8.2005.

**ಪ್ರಸ್ತಾವನೆ:**

ಮೇಲೆ ಓದಲಾಗಿರುವ ಸರ್ಕಾರದ ಪತ್ರದಲ್ಲಿ 2005ರ ಮಾಹಿತಿ ಹಕ್ಕು ಕಾಯ್ದೆಯ ಸೆಕ್ಷನ್ 5(1) ರಡಿಯಲ್ಲಿ ಕರ್ನಾಟಕ ರಾಜ್ಯ ಗ್ರಾಹಕರ ವ್ಯಾಜ್ಯಗಳ ಪರಿಹಾರ ಆಯೋಗ ಮತ್ತು ಜಿಲ್ಲಾ ವೇದಿಕೆಗಳ ಸೇವೆಗೆ ಸಂಬಂಧಿಸಿದಂತೆ ಸಾರ್ವಜನಿಕ ಮಾಹಿತಿ ಅಧಿಕಾರಿ, ಕಲಂ 5(2) ರಡಿಯಲ್ಲಿ ಸಹಾಯಕ ಸಾರ್ವಜನಿಕ ಮಾಹಿತಿ ಅಧಿಕಾರಿ ಮತ್ತು ಕಲಂ 19(1) ರಡಿಯಲ್ಲಿ ಮೇಲ್ಮನವಿ ಪ್ರಾಧಿಕಾರ ಕುರಿತು ನೇಮಕ ಮಾಡುವಂತೆ ಕೋರಿರುವುದನ್ನು ಪರಿಶೀಲಿಸುತ್ತಾ ಈ ಕೆಳಕಂಡಂತೆ ಆದೇಶ ಮಾಡಲಾಗಿದೆ.

**ಆದೇಶ ಸಂಖ್ಯೆ: ಕರಾಅ:ಆಡಳಿತ:92:2000-01, ದಿನಾಂಕ: 29ನೇ ಆಗಸ್ಟ್ 2005**

2005ರ ಮಾಹಿತಿ ಹಕ್ಕು ಕಾಯ್ದೆ (2005ರ ಕಾಯ್ದೆ ಸಂಖ್ಯೆ 22) ಸೆಕ್ಷನ್ 19(1) ರಡಿಯಲ್ಲಿ ಕರ್ನಾಟಕ ರಾಜ್ಯ ಗ್ರಾಹಕರ ವ್ಯಾಜ್ಯಗಳ ಪರಿಹಾರ ಆಯೋಗದ ಮಾನ್ಯ ಅಧ್ಯಕ್ಷರನ್ನು ಮೇಲ್ಮನವಿ ಪ್ರಾಧಿಕಾರವೆಂದೂ, ಕಲಂ 5(1) ರಡಿಯಲ್ಲಿ ರಾಜ್ಯ ಆಯೋಗದ ರಿಜಿಸ್ಟ್ರಾರ್ ಮತ್ತು ಆಡಳಿತಾಧಿಕಾರಿಗಳನ್ನು "ಸಾರ್ವಜನಿಕ ಮಾಹಿತಿ ಅಧಿಕಾರಿ"ಯೆಂದು ಮತ್ತು ಕಲಂ 5(2) ರಡಿಯಲ್ಲಿ ರಾಜ್ಯ ಆಯೋಗದ ಶಿರಸ್ತೇದಾರ್‌ರವರನ್ನು ಸಹಾಯಕ ಸಾರ್ವಜನಿಕ ಮಾಹಿತಿ ಅಧಿಕಾರಿಯೆಂದು ಈ ಮೂಲಕ ನೇಮಕ ಮಾಡಲಾಗಿದೆ.

ಇದೇ ರೀತಿ ಸೆಕ್ಷನ್ 19(1) ರಡಿಯಲ್ಲಿ ಆಯಾ ಜಿಲ್ಲಾ ವೇದಿಕೆಗಳಿಗೆ ಸಂಬಂಧಿಸಿದಂತೆ ಜಿಲ್ಲಾ ವೇದಿಕೆಯ ಅಧ್ಯಕ್ಷರನ್ನು "ಮೇಲ್ಮನವಿ ಪ್ರಾಧಿಕಾರ"ವೆಂದು, ಸೆಕ್ಷನ್ 5(1) ರಡಿಯಲ್ಲಿ ಆಯಾಯ ಜಿಲ್ಲಾ ವೇದಿಕೆಗಳ ಸಹಾಯ ರಿಜಿಸ್ಟ್ರಾರ್ ಮತ್ತು ಸಹಾಯಕ ಆಡಳಿತಾಧಿಕಾರಿಗಳನ್ನು "ಸಾರ್ವಜನಿಕ ಮಾಹಿತಿ ಅಧಿಕಾರಿ" ಎಂದು ಮತ್ತು ಆಯಾ ಜಿಲ್ಲಾ ವೇದಿಕೆಗಳ ಶಿರಸ್ತೇದಾರ್‌ರವರನ್ನು "ಸಹಾಯಕ ಸಾರ್ವಜನಿಕ ಮಾಹಿತಿ ಅಧಿಕಾರಿ"ಯೆಂದು ಈ ಮೂಲಕ ನೇಮಕ ಮಾಡಲಾಗಿದೆ.

**ನ್ಯಾಯಮೂರ್ತಿ ಚಂದ್ರಶೇಖರಯ್ಯ**

ಪಿ.ಆರ್. 1237 ಕರ್ನಾಟಕ ರಾಜ್ಯ ಗ್ರಾಹಕರ ವ್ಯಾಜ್ಯಗಳ ಪರಿಹಾರ ಆಯೋಗ, ಬೆಂಗಳೂರು.

**ಪೊಲೀಸ್ ಕಮೀಷನರ್ ರವರ ಕಛೇರಿ, ನಂ.1, ಇನ್ ಫೆಂಟ್ರಿ ರಸ್ತೆ, ಬೆಂಗಳೂರು ನಗರ,**

**ಅಧಿಸೂಚನೆ ಸಂಖ್ಯೆ.17/ಸಂವಿ/ಸಿ.ಓ.ಪಿ/2005 ದಿನಾಂಕ: 20ನೇ ಆಗಸ್ಟ್ 2005**

ಬೆಂಗಳೂರು ನಗರ - ಹಲಸೂರು ಸಂಚಾರ ಪೊಲೀಸ್ ಠಾಣೆ ಸರಹದ್ದಿನ ಬ್ರಂಟನ್ ರಸ್ತೆಯು ಎಂ.ಜಿ. ರಸ್ತೆ ಜಂಕ್ಷನ್‌ನಿಂದ ಬ್ರಂಟನ್ ರಸ್ತೆ ಕ್ರಾಸ್ ವರೆಗೆ ಎರಡೂ ಕಡೆಗಳಲ್ಲಿ ಪ್ರತಿಷ್ಠಿತ ಹೋಟೆಲ್‌ಗಳು, ಸಾಫ್ಟ್‌ವೇರ್ ಕಂಪನಿಗಳು ಹಾಗೂ ಪಾಸ್‌ಪೋರ್ಟ್ ಕಛೇರಿ ಇರುತ್ತವೆ. ಈ ರಸ್ತೆಯು ಕಿರಿದಾಗಿದ್ದು, ಪಾದಚಾರಿ ರಸ್ತೆಯನ್ನು ಹೊಂದಿರುವುದಿಲ್ಲ. ಈ ರಸ್ತೆಯಲ್ಲಿ ದ್ವಿಮುಖ ಸಂಚಾರ ವ್ಯವಸ್ಥೆ ಇದ್ದು, ಎರಡೂ ಕಡೆಯ ಬೃಹತ್ ಹೋಟೆಲ್‌ಗಳು ಹಾಗೂ ಕಟ್ಟಡ ಸಂಕೀರ್ಣಗಳ ಕಾರಣದಿಂದಾಗಿ ವಾಹನಗಳ ಸಂಚಾರ ಅಧಿಕವಾಗಿರುತ್ತದೆ. ಬ್ರಂಟನ್ ರಸ್ತೆಯಿಂದ ಬಂದ ವಾಹನಗಳು ಎಂ.ಜಿ. ರಸ್ತೆಗೆ ತಿರುವು ತೆಗೆದುಕೊಳ್ಳುವುದರಿಂದ ಈ ಜಾಗದಲ್ಲಿ ವಾಹನ ಸಂಚಾರ ಸ್ಥಗಿತಗೊಳ್ಳುತ್ತಿರುತ್ತದೆ. ಪ್ರಯುಕ್ತ ಬ್ರಂಟನ್ ರಸ್ತೆ-ಎಂ.ಜಿ. ರಸ್ತೆ ಕೂಡುವ ಜಂಕ್ಷನ್‌ನಲ್ಲಿನ ಸಂಚಾರ ಸ್ಥಗಿತವನ್ನು ತಹಬಂದಿಗೆ ತರುವ ಸಲುವಾಗಿ, ಬ್ರಂಟನ್ ರಸ್ತೆಯಲ್ಲಿ ಬ್ರಂಟನ್ ರಸ್ತೆ ಕ್ರಾಸ್ ಜಂಕ್ಷನ್‌ನಿಂದ ಎಂ.ಜಿ. ರಸ್ತೆ ಕಡೆಗೆ ಸಾಗುವ ಸಂಚಾರವನ್ನು ನಿರ್ಬಂಧಿಸಿ ಸುಗಮ ಸಂಚಾರಕ್ಕೆ ಅನುವು ಮಾಡಿಕೊಡುವುದು ಅವಶ್ಯಕವಾಗಿರುತ್ತದೆ.

ಆದ್ದರಿಂದ ಕಲಂ 115 ಮೋಟಾರ್ ವಾಹನ ಕಾಯ್ದೆ 1988 ಹಾಗೂ ಕಲಂ 3 ಕರ್ನಾಟಕ ಟ್ರಾಫಿಕ್ ಕಂಟ್ರೋಲ್ ಆಕ್ಟ್ 1960ರ ಪ್ರಕಾರ ನನಗೆ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ ಡಾ: ಅಜಯಕುಮಾರ ಸಿಂಹ, ಐ.ಪಿ.ಎಸ್, ಪೊಲೀಸ್ ಕಮೀಷನರ್, ಬೆಂಗಳೂರು ನಗರ ಆದ ನಾನು ಈ ಕೆಳಕಂಡಂತೆ ಸಂಚಾರ ನಿರ್ಬಂಧಗಳನ್ನು ಆದೇಶಿಸಿರುತ್ತೇನೆ.

"ಬ್ರಂಟನ್ ರಸ್ತೆಯಲ್ಲಿ ಬ್ರಂಟನ್ ರಸ್ತೆ ಕ್ರಾಸ್‌ನಿಂದ ಎಂ.ಜಿ. ರಸ್ತೆ ಜಂಕ್ಷನ್‌ವರೆಗಿನ ದ್ವಿಮುಖ ಸಂಚಾರ ವ್ಯವಸ್ಥೆಯಲ್ಲಿ ಎಂ.ಜಿ. ರಸ್ತೆ ಜಂಕ್ಷನ್‌ನಿಂದ ಬ್ರಂಟನ್ ರಸ್ತೆ ಕ್ರಾಸ್ ಜಂಕ್ಷನ್‌ವರೆಗೆ ಉತ್ತರದಿಂದ ದಕ್ಷಿಣಕ್ಕೆ ಸಾಗುವ ಸಂಚಾರವನ್ನು ಯಥಾಸ್ಥಿತಿಯಲ್ಲಿ ಉಳಿಸಿಕೊಂಡು ವಿರುದ್ಧ ದಿಕ್ಕಿನ ಸಂಚಾರವನ್ನು ಅಂದರೆ ಬ್ರಂಟನ್ ರಸ್ತೆ ಕ್ರಾಸ್ ಜಂಕ್ಷನ್‌ನಿಂದ ಎಂ.ಜಿ. ರಸ್ತೆ-ಬ್ರಂಟನ್ ರಸ್ತೆ ಜಂಕ್ಷನ್‌ವರೆಗೆ ದಕ್ಷಿಣದಿಂದ ಉತ್ತರಕ್ಕೆ ಸಾಗುವ ಸಂಚಾರವನ್ನು ನಿಷೇಧಿಸಲಾಗಿದೆ"

ಅಂತೆಯೇ ಕಲಂ 116 ಮೋಟಾರ್ ವಾಹನ ಕಾಯ್ದೆ 1988 ಹಾಗೂ ಕಲಂ 4 ಕರ್ನಾಟಕ ಟ್ರಾಫಿಕ್ ಕಂಟ್ರೋಲ್ ಆಕ್ಟ್ 1960ರಲ್ಲಿ ಪ್ರದತ್ತವಾದ ಅಧಿಕಾರವನ್ನು ಉಪಯೋಗಿಸಿಕೊಂಡು ಮೇಲ್ಕಂಡ ನಿರ್ಬಂಧನೆಯನ್ನು ಜಾರಿಗೊಳಿಸಲು ಬೇಕಾದ ಅಗತ್ಯ ಸೂಚನಾ ಫಲಕಗಳನ್ನು ಸೂಕ್ತ ಸ್ಥಳಗಳಲ್ಲಿ ಅಳವಡಿಸಲು ಸ್ಥಳೀಯ ಅಧಿಕಾರಿಗಳಿಗೆ ಆದೇಶಿಸಿರುತ್ತೇನೆ.

ಈ ಮೇಲ್ಕಂಡ ವ್ಯವಸ್ಥೆಯನ್ನು ದಿನಾಂಕ: 27.8.2005 ರಿಂದ ಜಾರಿಗೆ ಬರುವಂತೆ ಆದೇಶಿಸಿರುತ್ತೇನೆ.

ಈ ಆದೇಶವನ್ನು ನಾನು ಈ ದಿನ ಅಂದರೆ ದಿನಾಂಕ: 20.8.2005 ರಂದು ನನ್ನ ಸಹಿ ಮತ್ತು ಮುದ್ರೆಯೊಂದಿಗೆ ನೀಡಿರುತ್ತೇನೆ.

**ಡಾ: ಅಜಯಕುಮಾರ ಸಿಂಹ**

ಪಿ.ಆರ್. 1239 ಪೊಲೀಸ್ ಕಮೀಷನರ್, ಬೆಂಗಳೂರು ನಗರ.

**ನೋಂದಣಿ ಮತ್ತು ಮುದ್ರಾಂಕ ಇಲಾಖೆ**

**ನೇಮಕಾತಿ ಆದೇಶ**

**ಜಿಲ್ಲಾ ನೋಂದಣಾಧಿಕಾರಿಗಳು, ಬಿಜಾಪುರ ಇವರ ನಡವಳಿಗಳು**

**ವಿಷಯ:** ನೋಂದಣಿ ಮತ್ತು ಮುದ್ರಾಂಕ ಇಲಾಖೆಯ ಬಿಜಾಪುರ ಜಿಲ್ಲೆಯಲ್ಲಿ ದ್ವಿತೀಯ ದರ್ಜೆ ಸಹಾಯಕರ ವೃಂದದಲ್ಲಿ ಗುರುತಿಸಲ್ಪಟ್ಟ ಬ್ಯಾಕ್‌ಲಾಗ್ ಹುದ್ದೆಗಳಲ್ಲಿ ದ್ವಿತೀಯ ದರ್ಜೆ ಸಹಾಯಕರನ್ನು ನೇಮಕ ಮಾಡಿಕೊಳ್ಳುವ ಬಗ್ಗೆ.

**ಉಲ್ಲೇಖ:** 1. ನೋಂದಣಿ ಮಹಾಪರಿವೀಕ್ಷಕರು ಮತ್ತು ಮುದ್ರಾಂಕಗಳ ಆಯುಕ್ತರು ಬೆಂಗಳೂರು ಇವರಿಗೆ ಈ ಕಛೇರಿಯಿಂದ ಬರೆದಿರುವ ಪತ್ರ ಸಂಖ್ಯೆ:ಜಿನೋಬಿ/ಸಿಬ್ಬಂದಿ:5-1:2001-02/4326 ದಿನಾಂಕ: 15.1.2002.

2. ಸರ್ಕಾರದ ಅಧಿಸೂಚನೆ ಸಂಖ್ಯೆ: ಡಿಪಿಎಆರ್ 13 ಎಸ್‌ಬಿಸಿ 2001 ದಿನಾಂಕ: 21.11.2001 ರನ್ವಯ ಪ್ರಕಟಿಸಿರುವ ಕೆ.ಸಿ.ಎಸ್. (ಪರಿಶಿಷ್ಟ ಜಾತಿ ಮತ್ತು ಪರಿಶಿಷ್ಟ ಪಂಗಡದವರಿಗೆ ಮೀಸಲಿಟ್ಟು ತುಂಬದೇ ಇರುವ ಹುದ್ದೆಗಳ) ವಿಶೇಷ ನೇಮಕಾತಿ ನಿಯಮಗಳು 2001.
3. ನೋಂದಣಿ ಮಹಾಪರಿವೀಕ್ಷಕರು ಮತ್ತು ಮುದ್ರಾಂಕಗಳ ಆಯುಕ್ತರು ಬೆಂಗಳೂರು ಇವರ ಅಧಿಸೂಚನೆ ಸಂಖ್ಯೆ: EST-1-273/2001-02 ದಿನಾಂಕ: 1.8.2002 (ದಿನಾಂಕ: 8.8.2002 ರ ರಾಜ್ಯಪತ್ರದಲ್ಲಿ ಪ್ರಕಟವಾಗಿದೆ)
4. ನೋಂದಣಿ ಮಹಾಪರಿವೀಕ್ಷಕರು ಮತ್ತು ಮುದ್ರಾಂಕಗಳ ಆಯುಕ್ತರು, ಬೆಂಗಳೂರು ಇವರ ಅಂತಿಮ ಆಯ್ಕೆ ಪಟ್ಟಿ ಸಂಖ್ಯೆ EST-1-273/2001-02 ದಿನಾಂಕ: 23.11.2004
5. ನೋಂದಣಿ ಮಹಾಪರಿವೀಕ್ಷಕರು ಮತ್ತು ಮುದ್ರಾಂಕಗಳ ಆಯುಕ್ತರು, ಬೆಂಗಳೂರು ಇವರ ಅಲಾಟ್‌ಮೆಂಟ್ ಆದೇಶ ಸಂಖ್ಯೆ: EST-1-273/2001-02 ದಿನಾಂಕ: 6.8.2005

**ಪ್ರಸ್ತಾವನೆ:**

ಈ ಇಲಾಖೆಯ ಬಿಜಾಪುರ ಜಿಲ್ಲೆಯಲ್ಲಿ ದ್ವಿತೀಯ ದರ್ಜೆ ಸಹಾಯಕರ ವೃಂದದಲ್ಲಿ ಕೆಳಕಂಡಂತೆ ಬ್ಯಾಕ್‌ಲಾಗ್ ಹುದ್ದೆಗಳು ಇರುತ್ತವೆಂದು ಈ ಕಛೇರಿಯಿಂದ ಉಲ್ಲೇಖ (1) ರನ್ವಯ ನೋಂದಣಿ ಮಹಾಪರಿವೀಕ್ಷಕರು ಮತ್ತು ಮುದ್ರಾಂಕಗಳು ಆಯುಕ್ತರು, ಬೆಂಗಳೂರು ಇವರಿಗೆ ವರದಿ ಮಾಡಲಾಗಿತ್ತು.

| ಕ್ರ. ಸಂ. | ಜಿಲ್ಲೆ | ಸದರಿ ಜಿಲ್ಲೆಯಲ್ಲಿ ಗುರುತಿಸಲ್ಪಟ್ಟ ಬ್ಯಾಕ್‌ಲಾಗ್ ಹುದ್ದೆಗಳ ಸಂಖ್ಯೆ | | |
|---|---|---|---|---|
| | | ಪರಿಶಿಷ್ಟ ಜಾತಿ | ಪರಿಶಿಷ್ಟ ಪಂಗಡ | ಒಟ್ಟು |
| 1 | ಬಿಜಾಪುರ ಜಿಲ್ಲೆ | ಒಂದು | ಒಂದು | ಎರಡು |

ಈ ಬ್ಯಾಕ್‌ಲಾಗ್ ಹುದ್ದೆಗಳನ್ನು ನೇರ ನೇಮಕಾತಿ ಮೂಲಕ ಭರ್ತಿ ಮಾಡುವ ಸಲುವಾಗಿ ಉಲ್ಲೇಖ (2)ರ ಬ್ಯಾಕ್‌ಲಾಗ್ ನಿಯಮಗಳ ಪ್ರಕಾರ ನೋಂದಣಿ ಮಹಾ ಪರಿವೀಕ್ಷಕರು ಮತ್ತು ಮುದ್ರಾಂಕಗಳ ಆಯುಕ್ತರು ಬೆಂಗಳೂರು ಇವರು ಪರಿಶಿಷ್ಟ ಜಾತಿ ಮತ್ತು ಪರಿಶಿಷ್ಟ ಪಂಗಡದ ಅಭ್ಯರ್ಥಿಗಳಿಂದ ಉಲ್ಲೇಖ (3)ರ ಅಧಿಸೂಚನೆ ಮೂಲಕ ಅರ್ಜಿಗಳನ್ನು ಆಹ್ವಾನಿಸಿ, ಈ ಬಗ್ಗೆ ಸ್ವೀಕೃತವಾದ ಎಲ್ಲಾ ಅರ್ಜಿಗಳು ಪರಿಶೀಲನೆಗೊಂಡ ನಂತರ ಉಲ್ಲೇಖ (2)ರ ಬ್ಯಾಕ್‌ಲಾಗ್ ನಿಯಮಗಳ ಪ್ರಕಾರ 29 ರಿಂದ 40 ವರ್ಷ ವಯೋಮಿತಿಯಲ್ಲಿರುವ ಅರ್ಹ ಅಭ್ಯರ್ಥಿಗಳನ್ನು Merit ಮತ್ತು ಮೀಸಲಾತಿ ಆಧಾರದ ಮೇಲೆ ಆಯ್ಕೆ ಮಾಡಿ ಅರ್ಹ ಅಭ್ಯರ್ಥಿಗಳ ಅಂತಿಮ ಆಯ್ಕೆ ಪಟ್ಟಿಯನ್ನು ನಿಯಮಾನುಸಾರ ನೋಂದಣಿ ಮಹಾ ಪರಿವೀಕ್ಷಕರು ಮತ್ತು ಮುದ್ರಾಂಕಗಳ ಆಯುಕ್ತರು ಬೆಂಗಳೂರು ಇವರು ಉಲ್ಲೇಖ (4) ರನ್ವಯ ದಿನಾಂಕ: 23.11.2004 ರಂದು ಪ್ರಕಟಿಸಿ, ತದನಂತರ ಈ ಕಛೇರಿಯಿಂದ ಉಲ್ಲೇಖ (1)ರ ಪತ್ರದಲ್ಲಿ ಮೇಲ್ಕಂಡಂತೆ ವರದಿ ಮಾಡಿದ ಬ್ಯಾಕ್‌ಲಾಗ್ ಹುದ್ದೆಗಳಿಗೆ ಅನುಗುಣವಾಗಿ ಕೆಳಕಂಡ ಅಭ್ಯರ್ಥಿಯನ್ನು ನೋಂದಣಿ ಮಹಾ ಪರಿವೀಕ್ಷಕರು ಮತ್ತು ಮುದ್ರಾಂಕಗಳ ಆಯುಕ್ತರವರು ಉಲ್ಲೇಖ (5)ರ ಅವರ ಅಲಾಟ್‌ಮೆಂಟ್ ಆದೇಶದಲ್ಲಿ ಈ ಜಿಲ್ಲೆಗೆ ಅಲಾಟ್ ಮಾಡಿ ಸದರಿ ಅಭ್ಯರ್ಥಿಯನ್ನು ಈ ಜಿಲ್ಲೆಯಲ್ಲಿ ದ್ವಿತೀಯ ದರ್ಜೆ ಸಹಾಯಕರೆಂದು ನೇಮಕ ಮಾಡಿಕೊಳ್ಳುವಂತೆ ನಿರ್ದೇಶಿಸಿದ್ದರ ಮೇರೆ ಕೆಳಕಂಡ ಅಭ್ಯರ್ಥಿಯನ್ನು ಸದರಿ ಬ್ಯಾಕ್‌ಲಾಗ್ ಹುದ್ದೆಗಳಲ್ಲಿ ನೇಮಕ ಮಾಡಿಕೊಳ್ಳುವ ಸಲುವಾಗಿ ಕೆಳಕಂಡಂತೆ ಆದೇಶ ಹೊರಡಿಸಲಾಗಿದೆ.

**ಆದೇಶ**

**ಸಂಖ್ಯೆ:ಜಿನೋಂವಿ/ಸಿಬ್ಬಂದಿ/14/05-06, ದಿನಾಂಕ: 5ನೇ ಸೆಪ್ಟೆಂಬರ್ 2005**

ಪ್ರಸ್ತಾವನೆಯಲ್ಲಿ ವಿವರಿಸಿರುವ ಕಾರಣಗಳ ಹಿನ್ನೆಲೆಯಲ್ಲಿ ಹಾಗೂ ಉಲ್ಲೇಖ (2)ರ ಬ್ಯಾಕ್‌ಲಾಗ್ ನಿಯಮಗಳನ್ವಯ ಪ್ರದತ್ತವಾದ ಅಧಿಕಾರದ ಮೇರೆಗೆ ಉಲ್ಲೇಖ (5) ರಲ್ಲಿನ ಅಲಾಟ್‌ಮೆಂಟ್ ಆದೇಶದಲ್ಲಿ ಕಂಡು ಬಂದ ಕೆಳಕಂಡ ಅಭ್ಯರ್ಥಿಯನ್ನು ಈ ತಕ್ಷಣದಿಂದ ಜಾರಿಗೆ ಬರುವಂತೆ ಮತ್ತು ಮುಂದಿನ ಆದೇಶದವರೆಗೆ ಕೆಳಕಂಡ ಷರತ್ತುಗಳಿಗೆ ಒಳಪಡಿಸಿ ರೂ. 3000-75-3450-100-4450-125-5450 ರವೇತನ ಶ್ರೇಣಿಯಲ್ಲಿ ಇತರೆ ಭತ್ಯೆಗಳು ಸೇರಿದಂತೆ ತಾತ್ಕಾಲಿಕವಾಗಿ ದ್ವಿತೀಯ ದರ್ಜೆ ಸಹಾಯಕರೆಂದು ನೇಮಕ ಮಾಡಲಾಗಿದೆ. ಹಾಗೂ ಸದರಿ ಅಭ್ಯರ್ಥಿಯನ್ನು ಅವರ ಹೆಸರಿನ ಮುಂದೆ ಸೂಚಿಸಿರುವ ಕಛೇರಿಗೆ ದ್ವಿತೀಯ ದರ್ಜೆ ಸಹಾಯಕರೆಂದು ಸ್ಥಳ ನಿಯುಕ್ತಿಗೊಳಿಸಿದೆ.

| ಕ್ರ. ಸಂ. | ಅಭ್ಯರ್ಥಿಯ ಹೆಸರು ಮತ್ತು ವಿಳಾಸ | SC/ST | ಜನ್ಮ ದಿನಾಂಕ | 7.9.2002ರ ದಿನಾಂಕಕ್ಕೆ ಅಭ್ಯರ್ಥಿಯ ವಯಸ್ಸು ವ- ತಿಂ- ದಿ | ವಿದ್ಯಾರ್ಹತೆ ಮತ್ತು ಶೇಕಡಾವಾರು ಅಂಕಗಳು | ಅಭ್ಯರ್ಥಿಯನ್ನು ದ್ವಿತೀಯ ದರ್ಜೆ ಸಹಾಯಕರೆಂದು ನೇಮಕ ಮಾಡಿ ಸ್ಥಳ ನಿಯುಕ್ತಿಗೊಳಿಸಿದ ಕಛೇರಿ ಹೆಸರು | ಯಾವ ಮೀಸಲಾತಿ ಅಡಿಯಲ್ಲಿ ಮತ್ತು ಯಾವ ವರ್ಗೀಕರಣದ ಅಡಿಯಲ್ಲಿ ನೇಮಕ ಮಾಡಲಾಗಿದೆಯೋ ಅದರ ವಿವರ |
|---|---|---|---|---|---|---|---|
| 1. | ಶಾಂತಾ ಸೋಮಪ್ಪ ನಾಯಕ D/o ಸೋಮಪ್ಪ C/o ರಾಟು ಜವ್ಹಾಣ್ ಸಹಾಯಕ ಪ್ರಾಧ್ಯಾಪಕರು ಚವ್ಹಾಣ್ ಜ್ಯೂಸ್ ಸೆಂಟರ್, ಮೀನಾಕ್ಷಿ ಚೌಕ್ ಬಿಜಾಪುರ-586 101 | SC | 01.6.1969 | 33.3.06 | S.S.L.C. 71.000 | ಜಿಲ್ಲಾ ನೋಂದಣಿ ಕಛೇರಿ, ಬಿಜಾಪುರ, ಬಿಜಾಪುರ ಜಿಲ್ಲೆ | ಪರಿಶಿಷ್ಟ ಜಾತಿ ಮಹಿಳಾ ಅಭ್ಯರ್ಥಿ ಮುಖ್ಯಪಟ್ಟಿ |

S.S.L.C. ಅಂಕಪಟ್ಟಿಯ ನೋಂದಣಿ ಸಂಖ್ಯೆ: 177823/April 1985 (ವರ್ಷ) ದ ಪ್ರಕಾರ ಸದರಿ ಅಭ್ಯರ್ಥಿಯ ಜನ್ಮ ದಿನಾಂಕವು 1.6.1969 ಆಗಿರುತ್ತದೆ.

ಈ ನೇಮಕಾತಿ ಆದೇಶವು ಕೆಳಕಂಡ ಷರತ್ತುಗಳಿಗೆ ಒಳಪಟ್ಟಿರುತ್ತದೆ. ಮತ್ತು ಅಭ್ಯರ್ಥಿಗಳು ಈ ಷರತ್ತುಗಳಿಗೆ ಬದ್ಧರಾಗಿರತಕ್ಕದ್ದು.

ಷರತ್ತುಗಳು:

1. ಈ ನೇಮಕಾತಿಯು ತಾತ್ಕಾಲಿಕವಾಗಿದ್ದು ಸದರಿ ಅಭ್ಯರ್ಥಿಯನ್ನು ಯಾವುದೇ ನೋಟೀಸ್ ಅಥವಾ ಕಾರಣ ನೀಡದೇ ಯಾವುದೇ ಘಳಿಗೆಯಲ್ಲಾದರೂ ಕೆಲಸದಿಂದ ತೆಗೆದು ಹಾಕುವ ಷರತ್ತಿಗೆ ಒಳಪಟ್ಟು ನೇಮಕಾತಿ ಮಾಡಲಾಗಿದೆ.
2. ಸದರಿ ಅಭ್ಯರ್ಥಿಯನ್ನು ಕರ್ನಾಟಕ ನಾಗರೀಕ ಸೇವಾ (ಸಾಮಾನ್ಯ ನೇಮಕಾತಿ) ನಿಯಮಗಳು 1977 ರಲ್ಲಿನ ನಿಬಂಧನೆಗಳಿಗೆ ಒಳಪಡಿಸಿ ಮತ್ತು ಕರ್ತವ್ಯಕ್ಕೆ ಹಾಜರಾದ ದಿನಾಂಕದಿಂದ ಎರಡು ವರ್ಷದ ಅರ್ಹತಾ ಪರೀಕ್ಷಾ ಅವಧಿಗೆ ಒಳಪಡಿಸಿ ತಾತ್ಕಾಲಿಕವಾಗಿ ನೇಮಕ ಮಾಡಲಾಗಿದೆ.
3. ಈ ನೇಮಕಾತಿಯು ಆಗಿಂದಾಗ್ಗೆ ಜಾರಿಯಲ್ಲಿರುವ ಸೇವಾ ಷರತ್ತುಗಳು, ನಿಯಮ ಮತ್ತು ಆದೇಶಗಳಿಗೆ ಒಳಪಡುತ್ತದೆ. ಹಾಗೂ ಸದರಿ ಅಭ್ಯರ್ಥಿಗಳು ಕೆ.ಸಿ.ಎಸ್.ಆರ್. ಮತ್ತು ಕೆ.ಸಿ.ಎಸ್. (ನಡತೆ) ನಿಯಮಗಳು 1966 ರಲ್ಲಿನ ಮತ್ತು ಕೆ.ಸಿ.ಎಸ್. (ಸಿ.ಸಿ.ಎ) ನಿಯಮಗಳು 1957 ರಲ್ಲಿನ ಹಾಗೂ ಆಗಿಂದಾಗ್ಗೆ ಜಾರಿಗೆ ಬರುವ ಹಾಗೂ ಜಾರಿಯಲ್ಲಿರುವ ಇತರೆ ಸೇವಾ ಷರತ್ತುಗಳಿಗೆ ಮತ್ತು ನಿಬಂಧನೆಗಳಿಗೆ ಒಳಪಡುತ್ತಾರೆ.
4. ಈ ಆದೇಶ ಮುಟ್ಟಿದ 15 (ಹದಿನೈದು) ದಿನಗಳ ಅವಧಿಯೊಳಗೆ ಅಭ್ಯರ್ಥಿಯು ಕೆಲಸಕ್ಕೆ ಹಾಜರಾಗತಕ್ಕದ್ದು. ಒಂದು ವೇಳೆ ನಿಗದಿತ ಅವಧಿಯೊಳಗೆ ಕೆಲಸಕ್ಕೆ ಹಾಜರಾಗದಿದ್ದಲ್ಲಿ ಈ ನೇಮಕಾತಿ ರದ್ದಾಗುವುದು ಹಾಗೂ ನೇಮಕಾತಿ ಬಗ್ಗೆ ಅಭ್ಯರ್ಥಿಯು ಯಾವ ಹಕ್ಕನ್ನೂ ಹೊಂದಿರುವುದಿಲ್ಲವೆಂದು ತಿಳಿಯತಕ್ಕದ್ದು.
5. ಅರ್ಹತಾ ಪರೀಕ್ಷಾ ಅವಧಿಯು ಎರಡು ವರ್ಷಗಳೆಂದು ನಿಗದಿಪಡಿಸಿದೆ. ಈ ಅವಧಿಯೊಳಗೆ 1974ರ ಕರ್ನಾಟಕ ನಾಗರೀಕ ಸೇವಾ (ಸೇವಾ ಮತ್ತು ಕನ್ನಡ ಭಾಷಾ ಪರೀಕ್ಷೆಗಳು) ನಿಯಮಾವಳಿಯಲ್ಲಿ ಈ ಇಲಾಖೆಯ ದ್ವಿತೀಯ ದರ್ಜೆ ಸಹಾಯಕರ ಹುದ್ದೆಗಳಿಗೆ ನಿಗದಿಪಡಿಸಿದ ಇಲಾಖಾ ಪರೀಕ್ಷೆಗಳಲ್ಲಿ ಅಭ್ಯರ್ಥಿಯು ಕಡ್ಡಾಯವಾಗಿ ತೇರ್ಗಡೆ ಹೊಂದತಕ್ಕದ್ದು. ಇದಕ್ಕೆ ತಪ್ಪಿದಲ್ಲಿ ಕೆ.ಸಿ.ಎಸ್. (ಪ್ರೊಬೇಷನ್) ರೂಲ್ಸ್ 1977ರ ಅಡಿಯಲ್ಲಿ ಕಟ್ಟುನಿಟ್ಟಿನ ಕ್ರಮ ಜರುಗಿಸಲಾಗುವುದು.
6. ಅಭ್ಯರ್ಥಿಯು ತಮಗೆ ವಹಿಸಿದ ಕೆಲಸ ಕಾರ್ಯಗಳನ್ನು ತೃಪ್ತಿಕರವಾಗಿ ಮಾಡತಕ್ಕದ್ದು.
7. ವಿದ್ಯಾರ್ಹತೆಯ ಬಗ್ಗೆ ಇರುವ ಮೂಲ ಪ್ರಮಾಣ ಪತ್ರಗಳನ್ನು ಹಾಜರಾಗುವ ಕಛೇರಿಯಲ್ಲಿ ಆ ಕಛೇರಿಯ ಮುಖ್ಯಸ್ಥರ ಮುಂದೆ ಹಾಜರುಪಡಿಸತಕ್ಕದ್ದು.
8. ಜನ್ಮ ದಿನಾಂಕದ ಬಗ್ಗೆ ಮೂಲ ಪ್ರಮಾಣ ಪತ್ರವನ್ನು ಹಾಜರಾಗುವ ಕಛೇರಿಯಲ್ಲಿ ಆ ಕಛೇರಿಯ ಮುಖ್ಯಸ್ಥರ ಮುಂದೆ ಹಾಜರುಪಡಿಸತಕ್ಕದ್ದು.
9. ಭಾರತದ ಸಂವಿಧಾನಕ್ಕೆ ಬದ್ಧರಾಗಿರುವ ಬಗ್ಗೆ ನಿಷ್ಠೆ ಪ್ರಮಾಣ ಪತ್ರವನ್ನು (ಪ್ರತಿಜ್ಞಾ ವಿಧಿ) ಬರೆದುಕೊಡತಕ್ಕದ್ದು.
10. ಕೆಲಸಕ್ಕೆ ಹಾಜರಾಗುವ ಮುನ್ನ ಅಭ್ಯರ್ಥಿಯು ಸಂಬಂಧಪಟ್ಟ ಜಿಲ್ಲಾ ಸರ್ಜನ್‌ನಿಂದ ದೈಹಿಕ ಪ್ರಮಾಣ ಪತ್ರವನ್ನು ನಿಗದಿತ ನಮೂನೆಯಲ್ಲಿ ಪಡೆದು ಹಾಜರಾಗುವ ಕಛೇರಿಯಲ್ಲಿ ಆ ಕಛೇರಿಯ ಮುಖ್ಯಸ್ಥರ ಮುಂದೆ ಹಾಜರುಪಡಿಸತಕ್ಕದ್ದು.
11. ಅಭ್ಯರ್ಥಿಯು ಕಡೆಯದಾಗಿ ಹಾಜರಾಗಿದ್ದ ಶಾಲೆಯ ಮುಖ್ಯೋಪಾಧ್ಯಾಯರು ನೀಡಿರುವ ನಡತೆ ಪ್ರಮಾಣ ಪತ್ರವನ್ನು ಹಾಜರಾಗುವ ಕಛೇರಿಯಲ್ಲಿ ಆ ಕಛೇರಿಯ ಮುಖ್ಯಸ್ಥರ ಮುಂದೆ ಹಾಜರುಪಡಿಸತಕ್ಕದ್ದು.
12. ಅಭ್ಯರ್ಥಿಯು ಮದುವೆಯಾಗಿದ್ದಲ್ಲಿ ಒಬ್ಬರೇ ಪತಿ ಅಥವಾ ಪತ್ನಿ ಹೊಂದಿರುವ ಬಗ್ಗೆ ಕೆ.ಸಿ.ಎಸ್. (ನಡತೆ) ನಿಯಮಗಳು 1966 ರಲ್ಲಿನ ನಿಯಮ 28ರ ರೀತ್ಯಾ ಹಾಜರಾಗುವ ಕಛೇರಿಯಲ್ಲಿ ಆ ಕಛೇರಿಯ ಮುಖ್ಯಸ್ಥರ ಮುಂದೆ ಘೋಷಣೆ ಹಾಜರ್‌ಪಡಿಸತಕ್ಕದ್ದು.
13. ಅಭ್ಯರ್ಥಿಯು ತಮ್ಮ ಜಾತಿ, ಜನ್ಮ ದಿನಾಂಕ, ವಿದ್ಯಾರ್ಹತೆ ಇತ್ಯಾದಿಯಾಗಿ ಯಾವುದೇ ವಿಚಾರದಲ್ಲಿ ಅಭ್ಯರ್ಥಿಯು ನೀಡಿರುವ ವಿವರಗಳು ಸುಳ್ಳೆಂದಾಗಲೀ ಅಥವಾ ತಪ್ಪೆಂದಾಗಲೀ ತಿಳಿದು ಬಂದಲ್ಲಿ ಅಂತಹ ಅಭ್ಯರ್ಥಿಯ ವಿರುದ್ಧ ಭಾರತೀಯ ದಂಡ ಸಂಹಿತೆಯಲ್ಲಿನ ಸೂಕ್ತ ಕಲಂಗಳ ಅಡಿಯಲ್ಲಿ ಕ್ರಮ ಕೈಗೊಳ್ಳಲಾಗುವುದು. ಹಾಗೂ ಕೆ.ಸಿ.ಎಸ್ (ಸಿ.ಸಿ.ಎ) ನಿಯಮಗಳು 1957ರ ಅಡಿಯಲ್ಲಿ ಶಿಸ್ತು ಕ್ರಮ ಕೈಗೊಳ್ಳಲಾಗುವುದು.
14. ಮಹಿಳಾ ಮೀಸಲಾತಿ ಅಡಿಯಲ್ಲಿ ಆಯ್ಕೆಯಾದ ಎಲ್ಲಾ ಮಹಿಳಾ ಅಭ್ಯರ್ಥಿಗಳು ಗೌರವಾನ್ವಿತ ಭಾರತದ ಸರ್ವೋಚ್ಚ ನ್ಯಾಯಾಲಯದಲ್ಲಿ ದಾಖಲಾಗಿರುವ ರಿಟ್ ಅರ್ಜಿ (ಸಿವಿಲ್) ಸಂಖ್ಯೆ 232/99 (ಶ್ರೀ ಬಿ.ಎಲ್. ನಾರಾಯಣ - VS - ಕರ್ನಾಟಕ ರಾಜ್ಯ ಮತ್ತು ಇತರರು) ಇದರಲ್ಲಿ ಆಗುವ ಅಂತಿಮ ತೀರ್ಪಿಗೆ ಬದ್ಧರಾಗಿರತಕ್ಕದ್ದು ಹಾಗೂ ದ್ವಿತೀಯ ದರ್ಜೆ ಸಹಾಯಕರ ಹುದ್ದೆಯ ಮೇಲೆ ಯಾವುದೇ ಹಕ್ಕನ್ನು ಹೊಂದಿರತಕ್ಕದಲ್ಲ ಅಥವಾ ಯಾವುದೇ ಹಕ್ಕನ್ನು ಸಾಧಿಸತಕ್ಕದ್ದಲ್ಲವೆಂದು ತಿಳಿಯತಕ್ಕದ್ದು ಹಾಗೂ ಸದರಿ ರಿಟ್ ಅರ್ಜಿ (ಸಿವಿಲ್) ಸಂಖ್ಯೆ: 232 : 99 ರಲ್ಲಿ ಆಗುವ ಅಂತಿಮ ತೀರ್ಪಿಗೆ ಬದ್ಧಳಾಗಿರುತ್ತೇನೆ ಎಂಬ ಬಗ್ಗೆ 20/- ರೂ. ಗಳ ಛಾಪಾ ಕಾಗದದಲ್ಲಿ ಮುಚ್ಚಳಿಕೆ ನಮೂನೆ-3 ಅನ್ನು ಈ ಕಛೇರಿಗೆ ಬರೆದುಕೊಡತಕ್ಕದ್ದು.
15. ಅಭ್ಯರ್ಥಿಗಳು ಸಲ್ಲಿಸಿರುವ ಅಂಕಪಟ್ಟಿಗಳು ಮತ್ತು ಮೀಸಲಾತಿ ಪ್ರಮಾಣ ಪತ್ರಗಳು ಹಾಗೂ ಜಾತಿ ಪ್ರಮಾಣ ಪತ್ರಗಳು ಸಕ್ಷಮ ಪ್ರಾಧಿಕಾರದಿಂದ ಸತ್ಯಾಪನೆಗೆ ಒಳಪಡುತ್ತವೆ.
16. ಒಂದು ವೇಳೆ ಅಭ್ಯರ್ಥಿಯು ಸಲ್ಲಿಸಿರುವ ಅಂಕಪಟ್ಟಿಗಳು ಮತ್ತು ಮೀಸಲಾತಿ ಪ್ರಮಾಣ ಪತ್ರಗಳು ಹಾಗೂ ಜಾತಿ ಪ್ರಮಾಣ ಪತ್ರಗಳು ಸುಳ್ಳು ಅಥವಾ ನಕಲಿ ಎಂದು ದೃಢಪಟ್ಟಲ್ಲಿ ಅಂತಹ ಅಭ್ಯರ್ಥಿಗಳ ಆಯ್ಕೆಯನ್ನು ಮತ್ತು ನೇಮಕಾತಿಯನ್ನು ಶಾಶ್ವತವಾಗಿ ರದ್ದುಪಡಿಸಲಾಗುವುದು ಹಾಗೂ ಅಭ್ಯರ್ಥಿಯ ವಿರುದ್ಧ ಭಾರತೀಯ ದಂಡ ಸಂಹಿತೆಯಲ್ಲಿನ ಸೂಕ್ತ ಕಲಂಗಳ ಅಡಿಯಲ್ಲಿ ಕ್ರಮ ಕೈಗೊಳ್ಳಲಾಗುವುದು ಹಾಗೂ KCS (CCA) ನಿಯಮಗಳು 1957ರ ಅಡಿಯಲ್ಲಿ ಶಿಸ್ತು ಕ್ರಮ ಕೈಗೊಳ್ಳಲಾಗುವುದು. ಇದಕ್ಕೆ ಬದ್ಧನಾಗಿರುತ್ತೇನೆ ಎಂಬ ಬಗ್ಗೆ ಅಭ್ಯರ್ಥಿಯು 20/- ರೂಗಳ ಛಾಪಾ ಕಾಗದದಲ್ಲಿ ಮುಚ್ಚಳಿಕೆ ನಮೂನೆ-1 ಅನ್ನು ಈ ಕಛೇರಿಗೆ ಬರೆದುಕೊಡತಕ್ಕದ್ದು.
17. ಅಭ್ಯರ್ಥಿಗಳು ಪರಿಶಿಷ್ಟ ಜಾತಿ ಮತ್ತು ಪರಿಶಿಷ್ಟ ಪಂಗಡದ ಅಭ್ಯರ್ಥಿಗಳಲ್ಲವೆಂದು ಸತ್ಯಾಪನೆಯಿಂದ ದೃಢಪಟ್ಟಲ್ಲಿ ಅಂತಹ ಅಭ್ಯರ್ಥಿಗಳ ನೇಮಕಾತಿಯನ್ನು ಶಾಶ್ವತವಾಗಿ ಯಾವುದೇ ಸೂಚನೆ ಇಲ್ಲದೇ ರದ್ದುಪಡಿಸಲಾಗುವುದು.

18. ಗ್ರಾಮೀಣ ಮೀಸಲಾತಿ ಅಡಿಯಲ್ಲಿ ಆಯ್ಕೆಗೊಂಡ ಅಭ್ಯರ್ಥಿಗಳು ಗ್ರಾಮೀಣ ಅಭ್ಯರ್ಥಿಗಳಲ್ಲವೆಂದು ಹಾಗೂ ಮಾಜಿ ಸೈನಿಕರ ಮೀಸಲಾತಿಯಲ್ಲಿ ಆಯ್ಕೆಗೊಂಡವರು ಮಾಜಿ ಸೈನಿಕರಲ್ಲವೆಂದು ದೃಢಪಟ್ಟಲ್ಲಿ ಅಂತಹ ಅಭ್ಯರ್ಥಿಗಳ ನೇಮಕಾತಿಯನ್ನು ಶಾಶ್ವತವಾಗಿ ಯಾವುದೇ ಸೂಚನೆ ಇಲ್ಲದೇ ರದ್ದುಪಡಿಸಲಾಗುವುದು.
19. ಇದೇ ರೀತಿ ಯೋಜನಾ ನಿರಾಶ್ರಿತರ ಮೀಸಲಾತಿ ಅಡಿಯಲ್ಲಿ ಆಯ್ಕೆಗೊಂಡವರು ಯೋಜನಾ ನಿರಾಶ್ರಿತ ಅಭ್ಯರ್ಥಿಗಳಲ್ಲವೆಂದು ಮತ್ತು ಅಂಗವಿಕಲರ ಮೀಸಲಾತಿ ಅಡಿಯಲ್ಲಿ ಆಯ್ಕೆಗೊಂಡವರು ಅಂಗವಿಕಲ ಅಭ್ಯರ್ಥಿಗಳಲ್ಲವೆಂದು ದೃಢಪಟ್ಟಲ್ಲಿ ಅಂತಹ ಅಭ್ಯರ್ಥಿಗಳ ನೇಮಕಾತಿಯನ್ನು ಶಾಶ್ವತವಾಗಿ ಯಾವುದೇ ಸೂಚನೆ ಇಲ್ಲದೇ ರದ್ದುಪಡಿಸಲಾಗುವುದು.
20. ಈ ನೇಮಕಾತಿ ಆದೇಶವು ಯಾವುದೇ ಸಂದರ್ಭದಲ್ಲಾದರೂ ತಿದ್ದೋಲೆ ಮತ್ತು ಮಾರ್ಪಾಡಿಗೆ ಒಳಪಟ್ಟಿರುತ್ತದೆ.
21. ನೇಮಕಾತಿ ಮಾಡಿರುವ ಸ್ಥಳದ ಅಥವಾ ಕಛೇರಿಯ ಮಾರ್ಪಾಡಿಗಾಗಿ ಯಾವುದೇ ಮನವಿಗಳನ್ನು ಯಾವುದೇ ಕಾರಣಕ್ಕಾಗಲೀ ಪುರಸ್ಕರಿಸಲಾಗುವುದಿಲ್ಲ.
22. ಅಭ್ಯರ್ಥಿಯು KGID ಯಲ್ಲಿ ಸರ್ಕಾರಿ ವಿಮೆಯನ್ನು ಕಡ್ಡಾಯವಾಗಿ ಮಾಡತಕ್ಕದ್ದು.
23. ಈ ನೇಮಕಾತಿಗಾಗಿ ಅರ್ಜಿ ಸಲ್ಲಿಸಿರುವ ಅಭ್ಯರ್ಥಿಗಳ ಪೈಕಿ ಬೇರೆ ಇನ್ನಾವುದೇ ಅಭ್ಯರ್ಥಿಯು ಅವರ ಆಯ್ಕೆಯನ್ನು ದಾಖಲೆ ಸಹಿತ establish ಮಾಡಿದಲ್ಲಿ ಅಥವಾ ನನ್ನ ನೇಮಕಾತಿಯು ಅಸಿಂಧುವೆಂದು ದಾಖಲೆಗಳ ಸಹಿತ ಸಾಬೀತುಪಡಿಸಿದಲ್ಲಿ ನನ್ನ ನೇಮಕಾತಿಯನ್ನು ಯಾವುದೇ ಸೂಚನೆ ಇಲ್ಲದೇ ಶಾಶ್ವತವಾಗಿ ರದ್ದುಗೊಳಿಸಿ ನನ್ನ ಬದಲಿಗೆ ಬೇರೊಬ್ಬರನ್ನು ಆಯ್ಕೆ ಮಾಡಬಹುದು ಎಂಬ ಬಗ್ಗೆ ಅಭ್ಯರ್ಥಿಯು 20/- ರೂ ಛಾಪಾ ಕಾಗದದಲ್ಲಿ ಮುಚ್ಚಳಿಕೆ ನಮೂನೆ-2 ಅನ್ನು ಈ ಕಛೇರಿಗೆ ಬರೆದುಕೊಡತಕ್ಕದ್ದು.
24. ಎರಡು ವರ್ಷದ ಪರೀಕ್ಷಾರ್ಥ ಅವಧಿಯಲ್ಲಿ ಅಭ್ಯರ್ಥಿಗಳು ತಮ್ಮ ವರ್ಗಾವಣೆಗಾಗಿ ರಾಜಕೀಯ ಅಥವಾ ಇನ್ನಾವುದೇ ರೀತಿಯ ಒತ್ತಡ ತಂದಲ್ಲಿ ಅಂತಹವರ ವಿರುದ್ಧ ಕಾನೂನು ರೀತ್ಯಾ ಶಿಸ್ತು ಕ್ರಮ ಜರುಗಿಸಲಾಗುವುದು.

ಪಿ.ಆರ್. 1241 ನೇಮಕಾತಿ ಪ್ರಾಧಿಕಾರಿ ಹಾಗೂ ಜಿಲ್ಲಾ ನೋಂದಣಾಧಿಕಾರಿಗಳು, ಬಿಜಾಪುರ ಜಿಲ್ಲೆ, ಬಿಜಾಪುರ.

## ನೋಂದಣಿ ಮತ್ತು ಮುದ್ರಾಂಕ ಇಲಾಖೆ

## ನೇಮಕಾತಿ ಆದೇಶ

**ಜಿಲ್ಲಾ ನೋಂದಣಾಧಿಕಾರಿ ಮತ್ತು ಮುದ್ರಾಂಕಗಳ ಉಪ ಆಯುಕ್ತರು, ಮೈಸೂರು ಜಿಲ್ಲೆ, ಮೈಸೂರು ಇವರ ನಡವಳಿಗಳು**

**ವಿಷಯ:** ನೋಂದಣಿ ಮತ್ತು ಮುದ್ರಾಂಕ ಇಲಾಖೆಯ ಮೈಸೂರು ಜಿಲ್ಲೆಯಲ್ಲಿ ದ್ವಿತೀಯ ದರ್ಜೆ ಸಹಾಯಕರ ವೃಂದದಲ್ಲಿ ಗುರುತಿಸಲ್ಪಟ್ಟ ಬ್ಯಾಕ್‌ಲಾಗ್ ಹುದ್ದೆಗಳಲ್ಲಿ ದ್ವಿತೀಯ ದರ್ಜೆ ಸಹಾಯಕರನ್ನು ನೇಮಕ ಮಾಡಿಕೊಳ್ಳುವ ಬಗ್ಗೆ.

**ಉಲ್ಲೇಖ:**
1. ನೋಂದಣಿ ಮಹಾಪರಿವೀಕ್ಷಕರು ಮತ್ತು ಮುದ್ರಾಂಕಗಳ ಆಯುಕ್ತರು ಬೆಂಗಳೂರು ಇವರಿಗೆ ಈ ಕಛೇರಿಯಿಂದ ಬರೆದಿರುವ ಪತ್ರ ಸಂಖ್ಯೆ:ಸಿಬ್ಬಂದಿ-142/ಬ್ಯಾಕ್‌ಲಾಗ್/2001-02, ದಿನಾಂಕ: 8.1.2002.
2. ಸರ್ಕಾರದ ಅಧಿಸೂಚನೆ ಸಂಖ್ಯೆ: ಡಿಪಿಎಆರ್ 13 ಎಸ್‌ಬಿಸಿ 2001 ದಿನಾಂಕ: 21.11.2001 ರನ್ವಯ ಪ್ರಕಟಿಸಿರುವ ಕೆ.ಸಿ.ಎಸ್. (ಪರಿಶಿಷ್ಟ ಜಾತಿ ಮತ್ತು ಪರಿಶಿಷ್ಟ ಪಂಗಡದವರಿಗೆ ಮೀಸಲಿಟ್ಟು ತುಂಬದೇ ಇರುವ ಹುದ್ದೆಗಳ) ವಿಶೇಷ ನೇಮಕಾತಿ ನಿಯಮಗಳು 2001.
3. ನೋಂದಣಿ ಮಹಾಪರಿವೀಕ್ಷಕರು ಮತ್ತು ಮುದ್ರಾಂಕಗಳ ಆಯುಕ್ತರು ಬೆಂಗಳೂರು ಇವರ ಅಧಿಸೂಚನೆ ಸಂಖ್ಯೆ: EST-1-273/2001-02 ದಿನಾಂಕ: 1.8.2002 (ದಿನಾಂಕ: 8.8.2002 ರ ರಾಜ್ಯಪತ್ರದಲ್ಲಿ ಪ್ರಕಟವಾಗಿದೆ)
4. ನೋಂದಣಿ ಮಹಾಪರಿವೀಕ್ಷಕರು ಮತ್ತು ಮುದ್ರಾಂಕಗಳ ಆಯುಕ್ತರು, ಬೆಂಗಳೂರು ಇವರ ಅಂತಿಮ ಆಯ್ಕೆ ಪಟ್ಟಿ ಸಂಖ್ಯೆ EST-1-273/2001-02 ದಿನಾಂಕ: 23.11.2004
5. ನೋಂದಣಿ ಮಹಾಪರಿವೀಕ್ಷಕರು ಮತ್ತು ಮುದ್ರಾಂಕಗಳ ಆಯುಕ್ತರು, ಬೆಂಗಳೂರು ಇವರ ಅಲಾಟ್‌ಮೆಂಟ್ ಆದೇಶ ಸಂಖ್ಯೆ: EST-1-273/2001-02 ದಿನಾಂಕ: 6.8.2005

**ಪ್ರಸ್ತಾವನೆ:**

ಈ ಇಲಾಖೆಯ ಮೈಸೂರು ಜಿಲ್ಲೆಯಲ್ಲಿ ದ್ವಿತೀಯ ದರ್ಜೆ ಸಹಾಯಕರ ವೃಂದದಲ್ಲಿ ಕೆಳಕಂಡಂತೆ ಬ್ಯಾಕ್‌ಲಾಗ್ ಹುದ್ದೆಗಳು ಇರುತ್ತವೆಂದು ಈ ಕಛೇರಿಯಿಂದ ಉಲ್ಲೇಖ-1ರನ್ವಯ ನೋಂದಣಿ ಮಹಾಪರಿವೀಕ್ಷಕರು ಮತ್ತು ಮುದ್ರಾಂಕಗಳ ಆಯುಕ್ತರು, ಬೆಂಗಳೂರು ಇವರಿಗೆ ವರದಿ ಮಾಡಲಾಗಿತ್ತು.

| ಕ್ರ. ಸಂ. | ಜಿಲ್ಲೆ | ಸದರಿ ಜಿಲ್ಲೆಯಲ್ಲಿ ಗುರುತಿಸಲ್ಪಟ್ಟ ಬ್ಯಾಕ್‌ಲಾಗ್ ಹುದ್ದೆಗಳ ಸಂಖ್ಯೆ | | |
|---|---|---|---|---|
| | | ಪರಿಶಿಷ್ಟ ಜಾತಿ | ಪರಿಶಿಷ್ಟ ಪಂಗಡ | ಒಟ್ಟು |
| 1 | ಮೈಸೂರು ಜಿಲ್ಲೆ | ಮೂರು | ಒಂದು | ನಾಲ್ಕು |

ಈ ಬ್ಯಾಕ್‌ಲಾಗ್ ಹುದ್ದೆಗಳನ್ನು ನೇರ ನೇಮಕಾತಿ ಮೂಲಕ ಭರ್ತಿ ಮಾಡುವ ಸಲುವಾಗಿ ಉಲ್ಲೇಖ (2)ರ ಬ್ಯಾಕ್‌ಲಾಗ್ ನಿಯಮಗಳ ಪ್ರಕಾರ ನೋಂದಣಿ ಮಹಾ ಪರಿವೀಕ್ಷಕರು ಮತ್ತು ಮುದ್ರಾಂಕಗಳ ಆಯುಕ್ತರು, ಬೆಂಗಳೂರು ಇವರು ಪರಿಶಿಷ್ಟ ಪಂಗಡದ ಅಭ್ಯರ್ಥಿಗಳಿಂದ ಉಲ್ಲೇಖ (3)ರ ಅಧಿಸೂಚನೆ ಮೂಲಕ ಅರ್ಜಿಗಳನ್ನು ಆಹ್ವಾನಿಸಿ, ಈ ಬಗ್ಗೆ ಸ್ವೀಕೃತವಾದ ಎಲ್ಲಾ ಅರ್ಜಿಗಳು ಪರಿಶೀಲನೆಗೊಂಡ ನಂತರ ಉಲ್ಲೇಖ (2) ಬ್ಯಾಕ್‌ಲಾಗ್ ನಿಯಮಗಳ ಪ್ರಕಾರ 29 ರಿಂದ 40 ವರ್ಷ ವಯೋಮಿತಿಯಲ್ಲಿರುವ ಅರ್ಹ ಅಭ್ಯರ್ಥಿಗಳನ್ನು Merit ಮತ್ತು ಮೀಸಲಾತಿ ಆಧಾರದ ಮೇಲೆ ಆಯ್ಕೆ ಮಾಡಿ ಅರ್ಹ ಅಭ್ಯರ್ಥಿಗಳ ಅಂತಿಮ ಆಯ್ಕೆ ಪಟ್ಟಿಯನ್ನು ನಿಯಮಾನುಸಾರ ನೋಂದಣಿ ಮಹಾಪರಿವೀಕ್ಷಕರು ಮತ್ತು ಮುದ್ರಾಂಕಗಳ ಆಯುಕ್ತರು, ಬೆಂಗಳೂರು ಇವರು ಉಲ್ಲೇಖ (4) ರನ್ವಯ ದಿನಾಂಕ: 23.11.2004 ರಂದು ಪ್ರಕಟಿಸಿ, ತದನಂತರ ಈ ಕಛೇರಿಯಿಂದ ಉಲ್ಲೇಖ (1)ರ ಪತ್ರದಲ್ಲಿ ಮೇಲ್ಕಂಡಂತೆ ವರದಿ ಮಾಡಿ ಬ್ಯಾಕ್‌ಲಾಗ್ ಹುದ್ದೆಗಳಿಗೆ ಅನುಗುಣವಾಗಿ ಕೆಳಕಂಡ ಅಭ್ಯರ್ಥಿಯನ್ನು ನೋಂದಣಿ ಮಹಾಪರಿವೀಕ್ಷಕರು ಮತ್ತು ಮುದ್ರಾಂಕಗಳ ಆಯುಕ್ತರವರು ಉಲ್ಲೇಖ (5)ರ ಅವರ ಅಲಾಟ್‌ಮೆಂಟ್ ಆದೇಶದಲ್ಲಿ ಈ ಜಿಲ್ಲೆಗೆ ಅಲಾಟ್‌ಮೆಂಟ್ ಮಾಡಿ ಸದರಿ ಅಭ್ಯರ್ಥಿಯನ್ನು ಈ ಜಿಲ್ಲೆಯಲ್ಲಿ ದ್ವಿತೀಯ ದರ್ಜೆ ಸಹಾಯಕರೆಂದು ನೇಮಕ ಮಾಡಿಕೊಳ್ಳುವಂತೆ ನಿರ್ದೇಶಿಸಿದ್ದರ ಮೇರೆ ಕೆಳಕಂಡ ಅಭ್ಯರ್ಥಿಯನ್ನು ಸದರಿ ಬ್ಯಾಕ್‌ಲಾಗ್ ಹುದ್ದೆಗಳಲ್ಲಿ ನೇಮಕ ಮಾಡಿಕೊಳ್ಳುವ ಸಲುವಾಗಿ ಕೆಳಕಂಡಂತೆ ಆದೇಶ ಹೊರಡಿಸಲಾಗಿದೆ.

## ಆದೇಶ

**ಸಂಖ್ಯೆ:ಸಿಬ್ಬಂದಿ.ಸಿಆರ್-142/2001-02, ದಿನಾಂಕ: 22ನೇ ಆಗಸ್ಟ್ 2005**

ಪ್ರಸ್ತಾವನೆಯಲ್ಲಿ ವಿವರಿಸಿರುವ ಕಾರಣಗಳ ಹಿನ್ನೆಲೆಯಲ್ಲಿ ಹಾಗೂ ಉಲ್ಲೇಖ (2)ರ ಬ್ಯಾಕ್‌ಲಾಗ್ ನಿಯಮಗಳನ್ವಯ ಪ್ರದತ್ತವಾದ ಅಧಿಕಾರದ ಮೇರೆಗೆ ಉಲ್ಲೇಖ (5) ರಲ್ಲಿನ ಅಲಾಟ್‌ಮೆಂಟ್ ಆದೇಶದಲ್ಲಿ ಕಂಡು ಬಂದ ಕೆಳಕಂಡ ಅಭ್ಯರ್ಥಿಯನ್ನು ಈ ತಕ್ಷಣದಿಂದ ಜಾರಿಗೆ ಬರುವಂತೆ ಮತ್ತು ಮುಂದಿನ ಆದೇಶದವರೆಗೆ ಕೆಳಕಂಡ ಷರತ್ತುಗಳಿಗೆ ಒಳಪಡಿಸಿ ರೂ. 3000-75-3450-100-4450-125-5450ರ ವೇತನ ಶ್ರೇಣಿಯಲ್ಲಿ ಇತರೆ ಭತ್ಯೆಗಳು ಸೇರಿದಂತೆ ತಾತ್ಕಾಲಿಕವಾಗಿ ದ್ವಿತೀಯ ದರ್ಜೆ ಸಹಾಯಕರೆಂದು ನೇಮಕ ಮಾಡಲಾಗಿದೆ. ಹಾಗೂ ಸದರಿ ಅಭ್ಯರ್ಥಿಯನ್ನು ಅವರ ಹೆಸರಿನ ಮುಂದೆ ಸೂಚಿಸಿರುವ ಕಛೇರಿಗೆ ದ್ವಿತೀಯ ದರ್ಜೆ ಸಹಾಯಕರೆಂದು ಸ್ಥಳ ನಿಯುಕ್ತಿಗೊಳಿಸಿದೆ.

| ಕ್ರ. ಸಂ. | ಅಭ್ಯರ್ಥಿಯ ಹೆಸರು ಮತ್ತು ವಿಳಾಸ | SC/ST | ಜನ್ಮ ದಿನಾಂಕ | 7.9.2002ರ ದಿನಾಂಕಕ್ಕೆ ಅಭ್ಯರ್ಥಿಯ ವಯಸ್ಸು ವ- ತಿಂ- ದಿ | ವಿದ್ಯಾರ್ಹತೆ ಮತ್ತು ಶೇಕಡಾವಾರು ಅಂಕಗಳು | ಅಭ್ಯರ್ಥಿಯನ್ನು ದ್ವಿತೀಯ ದರ್ಜೆ ಸಹಾಯಕರೆಂದು ನೇಮಕ ಮಾಡಿ ಸ್ಥಳ ನಿಯುಕ್ತಿಗೊಳಿಸಿದ ಕಛೇರಿ ಹೆಸರು | ಯಾವ ಮೀಸಲಾತಿ ಅಡಿಯಲ್ಲಿ ಮತ್ತು ಯಾವ ವರ್ಗೀಕರಣದ ಅಡಿಯಲ್ಲಿ ನೇಮಕ ಮಾಡಲಾಗಿದೆಯೋ ಅದರ ವಿವರ |
|---|---|---|---|---|---|---|---|
| 1. | ಪೂರ್ಣಿಮಾ. ಎಂ. D/o ಮುದ್ದುಚಲುವಯ್ಯ ಈಶ್ವರಿ ನಿಲಯ, ನಂ. 594, 12ನೇ ಮೈನ್, 28ನೇ ಕ್ರಾಸ್, 1ನೇ ಹಂತ ಡಿ. ಬ್ಲಾಕ್, ಜೆ.ಪಿ. ನಗರ, ಮೈಸೂರು-570 008 | SC | 7.7.1973 | 29.02.00 | S.S.L.C. 69.000 | ಉಪನೋಂದಣಿ ಕಚೇರಿ, ಹೆಚ್.ಡಿ. ಕೋಟೆ ಮೈಸೂರು ಜಿಲ್ಲೆ. | ಪರಿಶಿಷ್ಟ ಜಾತಿ ಮಹಿಳಾ ಅಭ್ಯರ್ಥಿ ಹೆಚ್ಚುವರಿ ಪಟ್ಟಿ |

S.S.L.C. ಅಂಕಪಟ್ಟಿಯ ನೋಂದಣಿ ಸಂಖ್ಯೆ: 309206/April 1989 (ವರ್ಷ) ದ ಪ್ರಕಾರ ಸದರಿ ಅಭ್ಯರ್ಥಿಯ ಜನ್ಮ ದಿನಾಂಕವು 7.7.1973 ಆಗಿರುತ್ತದೆ.

ಈ ನೇಮಕಾತಿ ಆದೇಶವು ಕೆಳಕಂಡ ಷರತ್ತುಗಳಿಗೆ ಒಳಪಟ್ಟಿರುತ್ತದೆ. ಮತ್ತು ಅಭ್ಯರ್ಥಿಗಳು ಈ ಷರತ್ತುಗಳಿಗೆ ಬದ್ಧರಾಗಿರತಕ್ಕದ್ದು.

**ಷರತ್ತುಗಳು:**

1. ಈ ನೇಮಕಾತಿಯು ತಾತ್ಕಾಲಿಕವಾಗಿದ್ದು ಸದರಿ ಅಭ್ಯರ್ಥಿಯನ್ನು ಯಾವುದೇ ನೋಟೀಸ್ ಅಥವಾ ಕಾರಣ ನೀಡದೇ ಯಾವುದೇ ಘಳಿಗೆಯಲ್ಲಾದರೂ ಕೆಲಸದಿಂದ ತೆಗೆದು ಹಾಕುವ ಷರತ್ತಿಗೆ ಒಳಪಟ್ಟು ನೇಮಕಾತಿ ಮಾಡಲಾಗಿದೆ.
2. ಸದರಿ ಅಭ್ಯರ್ಥಿಯನ್ನು ಕರ್ನಾಟಕ ನಾಗರೀಕ ಸೇವಾ (ಸಾಮಾನ್ಯ ನೇಮಕಾತಿ) ನಿಯಮಗಳು 1977 ರಲ್ಲಿನ ನಿಬಂಧನೆಗಳಿಗೆ ಒಳಪಡಿಸಿ ಮತ್ತು ಕರ್ತವ್ಯಕ್ಕೆ ಹಾಜರಾದ ದಿನಾಂಕದಿಂದ ಎರಡು ವರ್ಷದ ಅರ್ಹತಾ ಪರೀಕ್ಷಾ ಅವಧಿಗೆ ಒಳಪಡಿಸಿ ತಾತ್ಕಾಲಿಕವಾಗಿ ನೇಮಕ ಮಾಡಲಾಗಿದೆ.
3. ಈ ನೇಮಕಾತಿಯು ಆಗಿಂದಾಗ್ಗೆ ಜಾರಿಯಲ್ಲಿರುವ ಸೇವಾ ಷರತ್ತುಗಳು, ನಿಯಮ ಮತ್ತು ಆದೇಶಗಳಿಗೆ ಒಳಪಡುತ್ತದೆ. ಹಾಗೂ ಸದರಿ ಅಭ್ಯರ್ಥಿಗಳು ಕೆ.ಸಿ.ಎಸ್.ಆರ್. ಮತ್ತು ಕೆ.ಸಿ.ಎಸ್. (ನಡತೆ) ನಿಯಮಗಳು 1966 ರಲ್ಲಿನ ಮತ್ತು ಕೆ.ಸಿ.ಎಸ್. (ಸಿ.ಸಿ.ಎ) ನಿಯಮಗಳು 1957 ರಲ್ಲಿನ ಹಾಗೂ ಆಗಿಂದಾಗ್ಗೆ ಜಾರಿಗೆ ಬರುವ ಹಾಗೂ ಜಾರಿಯಲ್ಲಿರುವ ಇತರೆ ಸೇವಾ ಷರತ್ತುಗಳಿಗೆ ಮತ್ತು ನಿಬಂಧನೆಗಳಿಗೆ ಒಳಪಡುತ್ತಾರೆ.
4. ಈ ಆದೇಶ ಮುಟ್ಟಿದ 15 (ಹದಿನೈದು) ದಿನಗಳ ಅವಧಿಯೊಳಗೆ ಅಭ್ಯರ್ಥಿಯು ಕೆಲಸಕ್ಕೆ ಹಾಜರಾಗತಕ್ಕದ್ದು. ಒಂದು ವೇಳೆ ನಿಗದಿತ ಅವಧಿಯೊಳಗೆ ಕೆಲಸಕ್ಕೆ ಹಾಜರಾಗದಿದ್ದಲ್ಲಿ ಈ ನೇಮಕಾತಿ ರದ್ದಾಗುವುದು ಹಾಗೂ ನೇಮಕಾತಿ ಬಗ್ಗೆ ಅಭ್ಯರ್ಥಿಯು ಯಾವ ಹಕ್ಕನ್ನೂ ತಿಳಿಯತಕ್ಕದ್ದು.
5. ಅರ್ಹತಾ ಪರೀಕ್ಷಾ ಅವಧಿಯು ಎರಡು ವರ್ಷಗಳೆಂದು ನಿಗದಿಪಡಿಸಿದೆ. ಈ ಅವಧಿಯೊಳಗೆ 1974ರ ಕರ್ನಾಟಕ ನಾಗರೀಕ ಸೇವಾ (ಸೇವಾ ಮತ್ತು ಕನ್ನಡ ಭಾಷಾ ಪರೀಕ್ಷೆಗಳು) ನಿಯಮಾವಳಿಯಲ್ಲಿ ಈ ಇಲಾಖೆಯ ದ್ವಿತೀಯ ದರ್ಜೆ ಸಹಾಯಕರ ಹುದ್ದೆಗಳಿಗೆ ನಿಗದಿಪಡಿಸಿದ ಇಲಾಖಾ ಪರೀಕ್ಷೆಗಳಲ್ಲಿ ಅಭ್ಯರ್ಥಿಯು ಕಡ್ಡಾಯವಾಗಿ ತೇರ್ಗಡೆ ಹೊಂದತಕ್ಕದ್ದು. ಇದಕ್ಕೆ ತಪ್ಪಿದಲ್ಲಿ ಕೆ.ಸಿ.ಎಸ್. (ಪ್ರೊಬೇಷನ್) ರೂಲ್ಸ್ 1977ರ ಅಡಿಯಲ್ಲಿ ಕಟ್ಟುನಿಟ್ಟಿನ ಕ್ರಮ ಜರುಗಿಸಲಾಗುವುದು.
6. ಅಭ್ಯರ್ಥಿಯು ತಮಗೆ ವಹಿಸಿದ ಕೆಲಸ ಕಾರ್ಯಗಳನ್ನು ತೃಪ್ತಿಕರವಾಗಿ ಮಾಡತಕ್ಕದ್ದು.
7. ವಿದ್ಯಾರ್ಹತೆಯ ಬಗ್ಗೆ ಇರುವ ಮೂಲ ಪ್ರಮಾಣ ಪತ್ರಗಳನ್ನು ಹಾಜರಾಗುವ ಕಛೇರಿಯಲ್ಲಿ ಆ ಕಛೇರಿಯ ಮುಖ್ಯಸ್ಥರ ಮುಂದೆ ಹಾಜರುಪಡಿಸತಕ್ಕದ್ದು.
8. ಜನ್ಮ ದಿನಾಂಕದ ಬಗ್ಗೆ ಮೂಲ ಪ್ರಮಾಣ ಪತ್ರವನ್ನು ಹಾಜರಾಗುವ ಕಛೇರಿಯಲ್ಲಿ ಆ ಕಛೇರಿಯ ಮುಖ್ಯಸ್ಥರ ಮುಂದೆ ಹಾಜರುಪಡಿಸತಕ್ಕದ್ದು.
9. ಭಾರತದ ಸಂವಿಧಾನಕ್ಕೆ ಬದ್ಧರಾಗಿರುವ ಬಗ್ಗೆ ನಿಷ್ಠೆ ಪ್ರಮಾಣ ಪತ್ರವನ್ನು (ಪ್ರತಿಜ್ಞಾ ವಿಧಿ) ಬರೆದುಕೊಡತಕ್ಕದ್ದು.
10. ಕೆಲಸಕ್ಕೆ ಹಾಜರಾಗುವ ಮುನ್ನ ಅಭ್ಯರ್ಥಿಯು ಸಂಬಂಧಪಟ್ಟ ಜಿಲ್ಲಾ ಸರ್ಜನ್‌ನಿಂದ ದೈಹಿಕ ಪ್ರಮಾಣ ಪತ್ರವನ್ನು ಹಾಜರಾಗುವ ಕಛೇರಿಯಲ್ಲಿ ಆ ಕಛೇರಿಯ ಮುಖ್ಯಸ್ಥರ ಮುಂದೆ ಹಾಜರುಪಡಿಸತಕ್ಕದ್ದು.
11. ಅಭ್ಯರ್ಥಿಯು ಕಡೆಯದಾಗಿ ಹಾಜರಾಗಿದ್ದ ಶಾಲೆಯ ಮುಖ್ಯೋಪಾಧ್ಯಾಯರು ನೀಡಿರುವ ನಡತೆ ಪ್ರಮಾಣ ಪತ್ರವನ್ನು ಹಾಜರಾಗುವ ಕಛೇರಿಯಲ್ಲಿ ಆ ಕಛೇರಿಯ ಮುಖ್ಯಸ್ಥರ ಮುಂದೆ ಹಾಜರುಪಡಿಸತಕ್ಕದ್ದು.

12. ಅಭ್ಯರ್ಥಿಯು ಮದುವೆಯಾಗಿದ್ದಲ್ಲಿ ಒಬ್ಬರೇ ಪತಿ ಅಥವಾ ಪತ್ನಿ ಹೊಂದಿರುವ ಬಗ್ಗೆ ಕೆ.ಸಿ.ಎಸ್. (ನಡತೆ) ನಿಯಮಗಳು 1966 ರಲ್ಲಿನ ನಿಯಮ 28 ರೀತ್ಯಾ ಹಾಜರಾಗುವ ಕಛೇರಿಯಲ್ಲಿ ಆ ಕಛೇರಿಯ ಮುಖ್ಯಸ್ಥರ ಮುಂದೆ ಘೋಷಣೆ ಹಾಜರ್‌ಪಡಿಸತಕ್ಕದ್ದು.
13. ಅಭ್ಯರ್ಥಿಯು ತಮ್ಮ ಜಾತಿ, ಜನ್ಮ ದಿನಾಂಕ, ವಿದ್ಯಾರ್ಹತೆ ಇತ್ಯಾದಿಯಾಗಿ ಯಾವುದೇ ವಿಚಾರದಲ್ಲಿ ಅಭ್ಯರ್ಥಿಯು ನೀಡಿರುವ ವಿವರಗಳು ಸುಳ್ಳೆಂದಾಗಲೀ ಅಥವಾ ತಪ್ಪೆಂದಾಗಲೀ ತಿಳಿದು ಬಂದಲ್ಲಿ ಅಂತಹ ಅಭ್ಯರ್ಥಿಯ ವಿರುದ್ಧ ಭಾರತೀಯ ದಂಡ ಸಂಹಿತೆಯಲ್ಲಿನ ಸೂಕ್ತ ಕಲಂಗಳ ಅಡಿಯಲ್ಲಿ ಕ್ರಮ ಕೈಗೊಳ್ಳಲಾಗುವುದು. ಹಾಗೂ ಕೆ.ಸಿ.ಎಸ್ (ಸಿ.ಸಿ.ಎ) ನಿಯಮಗಳು 1957ರ ಅಡಿಯಲ್ಲಿ ಶಿಸ್ತು ಕ್ರಮ ಕೈಗೊಳ್ಳಲಾಗುವುದು.
14. ಮಹಿಳಾ ಮೀಸಲಾತಿ ಅಡಿಯಲ್ಲಿ ಆಯ್ಕೆಯಾದ ಎಲ್ಲಾ ಮಹಿಳಾ ಅಭ್ಯರ್ಥಿಗಳು ಗೌರವಾನ್ವಿತ ಭಾರತದ ಸರ್ವೋಚ್ಛ ನ್ಯಾಯಾಲಯದಲ್ಲಿ ದಾಖಲಾಗಿರುವ ರಿಟ್ ಅರ್ಜಿ (ಸಿವಿಲ್) ಸಂಖ್ಯೆ 232/99 (ಶ್ರೀ ಬಿ.ಎಲ್. ನಾರಾಯಣ - VS - ಕರ್ನಾಟಕ ರಾಜ್ಯ ಮತ್ತು ಇತರರು) ಇದರಲ್ಲಿ ಆಗುವ ಅಂತಿಮ ತೀರ್ಪಿಗೆ ಬದ್ಧರಾಗಿರತಕ್ಕದ್ದು ಹಾಗೂ ದ್ವಿತೀಯ ದರ್ಜೆ ಸಹಾಯಕರ ಹುದ್ದೆಯ ಮೇಲೆ ಯಾವುದೇ ಹಕ್ಕನ್ನು ಹೊಂದಿರತಕ್ಕದಲ್ಲ ಅಥವಾ ಯಾವುದೇ ಹಕ್ಕನ್ನು ಸಾಧಿಸತಕ್ಕದ್ದಲ್ಲವೆಂದು ತಿಳಿಯತಕ್ಕದ್ದು ಹಾಗೂ ಸದರಿ ರಿಟ್ ಅರ್ಜಿ (ಸಿವಿಲ್) ಸಂಖ್ಯೆ: 232/99 ರಲ್ಲಿ ಆಗುವ ಅಂತಿಮ ತೀರ್ಪಿಗೆ ಬದ್ಧಳಾಗಿರುತ್ತೇನೆ ಎಂಬ ಬಗ್ಗೆ 20/- ರೂ. ಗಳ ಛಾಪಾ ಕಾಗದದಲ್ಲಿ ಮುಚ್ಚಳಿಕೆ ನಮೂನೆ-3 ಅನ್ನು ಈ ಕಛೇರಿಗೆ ಬರೆದುಕೊಡತಕ್ಕದ್ದು.
15. ಅಭ್ಯರ್ಥಿಗಳು ಸಲ್ಲಿಸಿರುವ ಅಂಕಪಟ್ಟಿಗಳು ಮತ್ತು ಮೀಸಲಾತಿ ಪ್ರಮಾಣ ಪತ್ರಗಳು ಹಾಗೂ ಜಾತಿ ಪ್ರಮಾಣ ಪತ್ರಗಳು ಸಕ್ಷಮ ಪ್ರಾಧಿಕಾರದಿಂದ ಸತ್ಯಾಪನೆಗೆ ಒಳಪಡುತ್ತವೆ.
16. ಒಂದು ವೇಳೆ ಅಭ್ಯರ್ಥಿಯು ಸಲ್ಲಿಸಿರುವ ಅಂಕಪಟ್ಟಿಗಳು ಮತ್ತು ಮೀಸಲಾತಿ ಪ್ರಮಾಣ ಪತ್ರಗಳು ಹಾಗೂ ಜಾತಿ ಪ್ರಮಾಣ ಪತ್ರಗಳು ಸುಳ್ಳು ಅಥವಾ ನಕಲಿ ಎಂದು ದೃಢಪಟ್ಟಲ್ಲಿ ಅಂತಹ ಅಭ್ಯರ್ಥಿಗಳ ಆಯ್ಕೆಯನ್ನು ಮತ್ತು ನೇಮಕಾತಿಯನ್ನು ಶಾಶ್ವತವಾಗಿ ರದ್ದುಪಡಿಸಲಾಗುವುದು ಹಾಗೂ ಅಭ್ಯರ್ಥಿಯ ವಿರುದ್ಧ ಭಾರತೀಯ ದಂಡ ಸಂಹಿತೆಯಲ್ಲಿನ ಸೂಕ್ತ ಕಲಂಗಳ ಅಡಿಯಲ್ಲಿ ಕ್ರಮ ಕೈಗೊಳ್ಳಲಾಗುವುದು ಹಾಗೂ ಕೆ.ಸಿ.ಎಸ್ (ಸಿ.ಸಿ.ಎ) ನಿಯಮಗಳು 1957ರ ಅಡಿಯಲ್ಲಿ ಶಿಸ್ತು ಕ್ರಮ ಕೈಗೊಳ್ಳಲಾಗುವುದು. ಇದಕ್ಕೆ ಬದ್ಧನಾಗಿರುತ್ತೇನೆ ಎಂಬ ಬಗ್ಗೆ ಅಭ್ಯರ್ಥಿಯು 20-00 ರೂಗಳ ಛಾಪಾ ಕಾಗದದಲ್ಲಿ ಮುಚ್ಚಳಿಕೆ ನಮೂನೆ-1 ಅನ್ನು ಈ ಕಛೇರಿಗೆ ಬರೆದುಕೊಡತಕ್ಕದ್ದು.
17. ಅಭ್ಯರ್ಥಿಗಳು ಪರಿಶಿಷ್ಟ ಜಾತಿ ಮತ್ತು ಪರಿಶಿಷ್ಟ ಪಂಗಡದ ಅಭ್ಯರ್ಥಿಗಳಲ್ಲವೆಂದು ಸತ್ಯಾಪನೆಯಿಂದ ದೃಢಪಟ್ಟಲ್ಲಿ ಅಂತಹ ಅಭ್ಯರ್ಥಿಗಳ ನೇಮಕಾತಿಯನ್ನು ಶಾಶ್ವತವಾಗಿ ಯಾವುದೇ ಸೂಚನೆ ಇಲ್ಲದೇ ರದ್ದುಪಡಿಸಲಾಗುವುದು.
18. ಗ್ರಾಮೀಣ ಮೀಸಲಾತಿ ಅಡಿಯಲ್ಲಿ ಆಯ್ಕೆಗೊಂಡ ಅಭ್ಯರ್ಥಿಗಳು ಗ್ರಾಮೀಣ ಅಭ್ಯರ್ಥಿಗಳಲ್ಲವೆಂದು ಹಾಗೂ ಮಾಜಿ ಸೈನಿಕರ ಮೀಸಲಾತಿಯಲ್ಲಿ ಆಯ್ಕೆಗೊಂಡವರು ಮಾಜಿ ಸೈನಿಕರಲ್ಲವೆಂದು ದೃಢಪಟ್ಟಲ್ಲಿ ಅಂತಹ ಅಭ್ಯರ್ಥಿಗಳ ನೇಮಕಾತಿಯನ್ನು ಶಾಶ್ವತವಾಗಿ ಯಾವುದೇ ಸೂಚನೆ ಇಲ್ಲದೇ ರದ್ದುಪಡಿಸಲಾಗುವುದು.
19. ಇದೇ ರೀತಿ ಯೋಜನಾ ನಿರಾಶ್ರಿತರ ಮೀಸಲಾತಿ ಅಡಿಯಲ್ಲಿ ಆಯ್ಕೆಗೊಂಡವರು ಯೋಜನಾ ನಿರಾಶ್ರಿತ ಅಭ್ಯರ್ಥಿಗಳಲ್ಲವೆಂದು ಮತ್ತು ಅಂಗವಿಕಲರ ಮೀಸಲಾತಿ ಅಡಿಯಲ್ಲಿ ಆಯ್ಕೆಗೊಂಡವರು ಅಂಗವಿಕಲ ಅಭ್ಯರ್ಥಿಗಳಲ್ಲವೆಂದು ದೃಢಪಟ್ಟಲ್ಲಿ ಅಂತಹ ಅಭ್ಯರ್ಥಿಗಳ ನೇಮಕಾತಿಯನ್ನು ಶಾಶ್ವತವಾಗಿ ಯಾವುದೇ ಸೂಚನೆ ಇಲ್ಲದೇ ರದ್ದುಪಡಿಸಲಾಗುವುದು.
20. ಈ ನೇಮಕಾತಿ ಆದೇಶವು ಯಾವುದೇ ಸಂದರ್ಭದಲ್ಲಾದರೂ ತಿದ್ದೋಲೆ ಮತ್ತು ಮಾರ್ಪಾಡಿಗೆ ಒಳಪಟ್ಟಿರುತ್ತದೆ.
21. ನೇಮಕಾತಿ ಮಾಡಿರುವ ಸ್ಥಳದ ಅಥವಾ ಕಛೇರಿಯ ಮಾರ್ಪಾಡಿಗಾಗಿ ಯಾವುದೇ ಮನವಿಗಳನ್ನು ಯಾವುದೇ ಕಾರಣಕ್ಕಾಗಲೀ ಪುರಸ್ಕರಿಸಲಾಗುವುದಿಲ್ಲ.
22. ಅಭ್ಯರ್ಥಿಯು KGID ಯಲ್ಲಿ ಸರ್ಕಾರಿ ವಿಮೆಯನ್ನು ಕಡ್ಡಾಯವಾಗಿ ಮಾಡತಕ್ಕದ್ದು.
23. ಈ ನೇಮಕಾತಿಗಾಗಿ ಅರ್ಜಿ ಸಲ್ಲಿಸಿರುವ ಅಭ್ಯರ್ಥಿಗಳ ಪೈಕಿ ಬೇರೆ ಇನ್ನಾವುದೇ ಅಭ್ಯರ್ಥಿಯು ಅವರ ಆಯ್ಕೆಯನ್ನು ದಾಖಲೆ ಸಹಿತ establish ಮಾಡಿದಲ್ಲಿ ಅಥವಾ ನನ್ನ ನೇಮಕಾತಿಯು ಅಸಿಂಧುವೆಂದು ದಾಖಲೆಗಳ ಸಹಿತ ಸಾಬೀತುಪಡಿಸಿದಲ್ಲಿ ನನ್ನ ನೇಮಕಾತಿಯನ್ನು ಯಾವುದೇ ಸೂಚನೆ ಇಲ್ಲದೇ ಶಾಶ್ವತವಾಗಿ ರದ್ದುಗೊಳಿಸಿ ನನ್ನ ಬದಲಿಗೆ ಬೇರೊಬ್ಬರನ್ನು ಆಯ್ಕೆ ಮಾಡಬಹುದು ಎಂಬ ಬಗ್ಗೆ ಅಭ್ಯರ್ಥಿಯು 20/- ರೂ ಛಾಪಾ ಕಾಗದದಲ್ಲಿ ಮುಚ್ಚಳಿಕೆ ನಮೂನೆ-2 ಅನ್ನು ಈ ಕಛೇರಿಗೆ ಬರೆದುಕೊಡತಕ್ಕದ್ದು.
24. ಎರಡು ವರ್ಷದ ಪರೀಕ್ಷಾರ್ಥ ಅವಧಿಯಲ್ಲಿ ಅಭ್ಯರ್ಥಿಗಳು ತಮ್ಮ ವರ್ಗಾವಣೆಗಾಗಿ ರಾಜಕೀಯ ಅಥವಾ ಇನ್ನಾವುದೇ ರೀತಿಯ ಒತ್ತಡ ತಂದಲ್ಲಿ ಅಂತಹವರ ವಿರುದ್ಧ ಕಾನೂನು ರೀತ್ಯಾ ಶಿಸ್ತು ಕ್ರಮ ಜರುಗಿಸಲಾಗುವುದು.

**ಮ. ಬಸವರಾಜು**

ಪಿ.ಆರ್. 1242 ನೇಮಕಾತಿ ಪ್ರಾಧಿಕಾರಿ ಹಾಗೂ ಜಿಲ್ಲಾ ನೋಂದಣಾಧಿಕಾರಿಗಳು, ಮೈಸೂರು ಜಿಲ್ಲೆ, ಮೈಸೂರು.

## ನೋಂದಣಿ ಮತ್ತು ಮುದ್ರಾಂಕ ಇಲಾಖೆ

## ನೇಮಕಾತಿ ಆದೇಶ

### ಜಿಲ್ಲಾ ನೋಂದಣಾಧಿಕಾರಿಗಳು, ಹಾಸನ ಇವರ ನಡವಳಿಗಳು

**ವಿಷಯ:** ನೋಂದಣಿ ಮತ್ತು ಮುದ್ರಾಂಕ ಇಲಾಖೆಯ ಹಾಸನ ಜಿಲ್ಲೆಯಲ್ಲಿ ದ್ವಿತೀಯ ದರ್ಜೆ ಸಹಾಯಕರ ವೃಂದದಲ್ಲಿ ಗುರುತಿಸಲ್ಪಟ್ಟ ಬ್ಯಾಕ್‌ಲಾಗ್ ಹುದ್ದೆಗಳಲ್ಲಿ ದ್ವಿತೀಯ ದರ್ಜೆ ಸಹಾಯಕರನ್ನು ನೇಮಕ ಮಾಡಿಕೊಳ್ಳುವ ಬಗ್ಗೆ.

**ಉಲ್ಲೇಖ:**
1. ನೋಂದಣಿ ಮಹಾಪರಿವೀಕ್ಷಕರು ಮತ್ತು ಮುದ್ರಾಂಕಗಳ ಆಯುಕ್ತರು ಬೆಂಗಳೂರು ಇವರಿಗೆ ಈ ಕಛೇರಿಯಿಂದ ಬರೆದಿರುವ ಪತ್ರ ಸಂಖ್ಯೆ:ಸಿಬ್ಬಂದಿ-124:2001-02, ದಿನಾಂಕ: 21.12.2001.
2. ಸರ್ಕಾರದ ಅಧಿಸೂಚನೆ ಸಂಖ್ಯೆ: ಡಿಪಿಎಆರ್ 13 ಎಸ್‌ಬಿಸಿ 2001 ದಿನಾಂಕ: 21.11.2001 ರನ್ವಯ ಪ್ರಕಟಿಸಿರುವ ಕೆ.ಸಿ.ಎಸ್. (ಪರಿಶಿಷ್ಟ ಜಾತಿ ಮತ್ತು ಪರಿಶಿಷ್ಟ ಪಂಗಡದವರಿಗೆ ಮೀಸಲಿಟ್ಟು ತುಂಬದೇ ಇರುವ ಹುದ್ದೆಗಳ) ವಿಶೇಷ ನೇಮಕಾತಿ ನಿಯಮಗಳು 2001.
3. ನೋಂದಣಿ ಮಹಾಪರಿವೀಕ್ಷಕರು ಮತ್ತು ಮುದ್ರಾಂಕಗಳ ಆಯುಕ್ತರು ಬೆಂಗಳೂರು ಇವರ ಅಧಿಸೂಚನೆ ಸಂಖ್ಯೆ: EST-1-273/2001-02 ದಿನಾಂಕ: 1.8.2002 (ದಿನಾಂಕ: 8.8.2002 ರ ರಾಜ್ಯಪತ್ರದಲ್ಲಿ ಪ್ರಕಟವಾಗಿದೆ)

4. ನೋಂದಣಿ ಮಹಾಪರಿವೀಕ್ಷಕರು ಮತ್ತು ಮುದ್ರಾಂಕಗಳ ಆಯುಕ್ತರು, ಬೆಂಗಳೂರು ಇವರ ಅಂತಿಮ ಆಯ್ಕೆ ಪಟ್ಟಿ ಸಂಖ್ಯೆ EST-1-273/2001-02 ದಿನಾಂಕ: 23.11.2004
5. ನೋಂದಣಿ ಮಹಾಪರಿವೀಕ್ಷಕರು ಮತ್ತು ಮುದ್ರಾಂಕಗಳ ಆಯುಕ್ತರು, ಬೆಂಗಳೂರು ಇವರ ಅಲಾಟ್‌ಮೆಂಟ್ ಆದೇಶ ಸಂಖ್ಯೆ: EST-1-273/2001-02 ದಿನಾಂಕ:14.12.2004
6. ಈ ಕಛೇರಿಯ ನೇಮಕಾತಿ ಆದೇಶ ಸಂಖ್ಯೆ:EST: 98/04-05, ದಿನಾಂಕ: 28.12.2005.
7. ಈ ಕಛೇರಿಯ ರದ್ದತಿ ಆದೇಶ ಸಂಖ್ಯೆ:EST: 98/04-05, ದಿನಾಂಕ: 18.3.2005.
8. ನೋಂದಣಿ ಮಹಾಪರಿವೀಕ್ಷಕರು ಮತ್ತು ಮುದ್ರಾಂಕಗಳ ಆಯುಕ್ತರು, ಬೆಂಗಳೂರು ಇವರ ರೀ-ಅಲಾಟ್‌ಮೆಂಟ್ ಆರ್ಡರ್ ಸಂಖ್ಯೆ: EST-1-273/01-02 ದಿನಾಂಕ: 6.8.2005

**ಪ್ರಸ್ತಾವನೆ:**

ಈ ಇಲಾಖೆಯ ಹಾಸನ ಜಿಲ್ಲೆಯಲ್ಲಿ ದ್ವಿತೀಯ ದರ್ಜೆ ಸಹಾಯಕರ ವೃಂದದಲ್ಲಿ ಕೆಳಕಂಡಂತೆ ಬ್ಯಾಕ್‌ಲಾಗ್ ಹುದ್ದೆಗಳು ಇರುತ್ತವೆಂದು ಈ ಕಛೇರಿಯಿಂದ ಉಲ್ಲೇಖ-1ರನ್ವಯ ನೋಂದಣಿ ಮಹಾಪರಿವೀಕ್ಷಕರು ಮತ್ತು ಮುದ್ರಾಂಕಗಳ ಆಯುಕ್ತರು, ಬೆಂಗಳೂರು ಇವರಿಗೆ ವರದಿ ಮಾಡಲಾಗಿತ್ತು.

| ಕ್ರ. ಸಂ. | ಜಿಲ್ಲೆ | ಸದರಿ ಜಿಲ್ಲೆಯಲ್ಲಿ ಗುರುತಿಸಲ್ಪಟ್ಟ ಬ್ಯಾಕ್‌ಲಾಗ್ ಹುದ್ದೆಗಳ ಸಂಖ್ಯೆ | | |
|---|---|---|---|---|
| | | ಪರಿಶಿಷ್ಟ ಜಾತಿ | ಪರಿಶಿಷ್ಟ ಪಂಗಡ | ಒಟ್ಟು |
| 1 | ಹಾಸನ ಜಿಲ್ಲೆ | ಒಂದು | ಇಲ್ಲ | ಒಂದು |

ಈ ಬ್ಯಾಕ್‌ಲಾಗ್ ಹುದ್ದೆಗಳನ್ನು ನೇರ ನೇಮಕಾತಿ ಮೂಲಕ ಭರ್ತಿ ಮಾಡುವ ಸಲುವಾಗಿ ಉಲ್ಲೇಖ (2)ರ ಬ್ಯಾಕ್‌ಲಾಗ್ ನಿಯಮಗಳ ಪ್ರಕಾರ ನೋಂದಣಿ ಮಹಾ ಪರಿವೀಕ್ಷಕರು ಮತ್ತು ಮುದ್ರಾಂಕಗಳ ಆಯುಕ್ತರು, ಬೆಂಗಳೂರು ಇವರು ಪರಿಶಿಷ್ಟ ಜಾತಿ ಮತ್ತು ಪರಿಶಿಷ್ಟ ಪಂಗಡದ ಅಭ್ಯರ್ಥಿಗಳಿಂದ ಉಲ್ಲೇಖ (3)ರ ಅಧಿಸೂಚನೆ ಮೂಲಕ ಅರ್ಜಿಗಳನ್ನು ಆಹ್ವಾನಿಸಿ, ಈ ಬಗ್ಗೆ ಸ್ವೀಕೃತವಾದ ಎಲ್ಲಾ ಅರ್ಜಿಗಳು ಪರಿಶೀಲನೆಗೊಂಡ ನಂತರ ಉಲ್ಲೇಖ (2)ರ ಬ್ಯಾಕ್‌ಲಾಗ್ ನಿಯಮಗಳ ಪ್ರಕಾರ 29 ರಿಂದ 40 ವರ್ಷ ವಯೋಮಿತಿಯಲ್ಲಿರುವ ಅರ್ಹ ಅಭ್ಯರ್ಥಿಗಳನ್ನು Merit ಮತ್ತು ಮೀಸಲಾತಿ ಆಧಾರದ ಮೇಲೆ ಆಯ್ಕೆ ಮಾಡಿ ಅರ್ಹ ಅಭ್ಯರ್ಥಿಗಳ ಅಂತಿಮ ಆಯ್ಕೆ ಪಟ್ಟಿಯನ್ನು ನಿಯಮಾನುಸಾರ ನೋಂದಣಿ ಮಹಾಪರಿವೀಕ್ಷಕರು ಮತ್ತು ಮುದ್ರಾಂಕಗಳ ಆಯುಕ್ತರು, ಬೆಂಗಳೂರು ಇವರು ಉಲ್ಲೇಖ (4) ರನ್ವಯ ದಿನಾಂಕ: 23.11.2004 ರಂದು ಪ್ರಕಟಿಸಿ, ತದನಂತರ ಈ ಕಛೇರಿಯಿಂದ ಉಲ್ಲೇಖ (1)ರ ಪತ್ರದಲ್ಲಿ ಮೇಲ್ಕಂಡಂತೆ ವರದಿ ಮಾಡಿದ ಬ್ಯಾಕ್‌ಲಾಗ್ ಹುದ್ದೆಗಳಿಗೆ ಅನುಗುಣವಾಗಿ ಕೆಳಕಂಡ ಅಭ್ಯರ್ಥಿಯನ್ನು ನೋಂದಣಿ ಮಹಾಪರಿವೀಕ್ಷಕರು ಮತ್ತು ಮುದ್ರಾಂಕಗಳ ಆಯುಕ್ತರವರು ಉಲ್ಲೇಖ (5)ರ ಅವರ ಅಲಾಟ್‌ಮೆಂಟ್ ಆದೇಶದಲ್ಲಿ ಈ ಜಿಲ್ಲೆಗೆ ಅಲಾಟ್ ಮಾಡಿ ಸದರಿ ಅಭ್ಯರ್ಥಿಯನ್ನು ಈ ಜಿಲ್ಲೆಯಲ್ಲಿ ದ್ವಿತೀಯ ದರ್ಜೆ ಸಹಾಯಕರೆಂದು ನೇಮಕ ಮಾಡಿಕೊಳ್ಳುವಂತೆ ನಿರ್ದೇಶಿಸಿದ್ದರ ಮೇರೆ ಕೆಳಕಂಡ ಅಭ್ಯರ್ಥಿಯನ್ನು ಉಪನೋಂದಣಿ ಕಚೇರಿ, ನುಗ್ಗೇಹಳ್ಳಿ ಇಲ್ಲಿಗೆ ಉಲ್ಲೇಖ (6)ರ ಈ ಕಛೇರಿಯ ನೇಮಕಾತಿ ಆದೇಶದಲ್ಲಿ ದ್ವಿತೀಯ ದರ್ಜೆ ಸಹಾಯಕರೆಂದು ನೇಮಕಾತಿ ಮಾಡಿದ್ದು, ಸದರಿ ಅಭ್ಯರ್ಥಿಯು ಈ ಕಛೇರಿಯ ಉಲ್ಲೇಖ (6)ರ ನೇಮಕಾತಿ ಆದೇಶವನ್ನು ದಿನಾಂಕ: 20.1.2005 ರಂದು ಸ್ವೀಕರಿಸಿದ್ದರೂ ಸಹ ಸದರಿಯವರು ನೇಮಕ ಮಾಡಿದ ಕಛೇರಿಯಲ್ಲಿ ಈ ತಹಲ್ ವರೆವಿಗೂ ಕೆಲಸಕ್ಕೆ ಹಾಜರಾಗದೇ ಇದ್ದ ಕಾರಣ ಉಲ್ಲೇಖ (6) ರನ್ವಯ ಈ ಕಛೇರಿಯಿಂದ ಇವರಿಗೆ ನೀಡಿದ ನೇಮಕಾತಿ ಆದೇಶವನ್ನು ಉಲ್ಲೇಖ (7) ರನ್ವಯ ಈ ಕಛೇರಿಯಿಂದ ರದ್ದುಪಡಿಸಲಾಯಿತು. ಹಾಗೂ ಈ ವಿಷಯವನ್ನು ನೋಂದಣಿ ಮಹಾಪರಿವೀಕ್ಷಕರು ಮತ್ತು ಮುದ್ರಾಂಕ ಆಯುಕ್ತರು, ಬೆಂಗಳೂರು ಇವರಿಗೂ ಹಾಗೂ ಸದರಿ ಅಭ್ಯರ್ಥಿಗೂ ತಿಳಿಸಲಾಯಿತು. ಉಲ್ಲೇಖ (7)ರ ಈ ಕಛೇರಿಯ ರದ್ದತಿ ಆದೇಶವನ್ನು ಕೆಳಕಂಡ ಅಭ್ಯರ್ಥಿಯು ದಿನಾಂಕ: 1.4.2005 ರಂದು ಪಡೆದಿರುತ್ತಾರೆ.

| | | |
|---|---|---|
| 1. | ಬಸಣ್ಣ ಸಂಗಣ್ಣ ಮಾದರ ಮುಕ್ಕಾಂ : ಪೋಸ್ಟ್ : ಪೀರಾಪುರ ತಾಲ್ಲೂಕು : ಮುದ್ದೇಬಿಹಾಳ | ಪರಿಶಿಷ್ಟ ಜಾತಿ ಗ್ರಾಮೀಣ ಅಭ್ಯರ್ಥಿ ಮುಖ್ಯಪಟ್ಟಿ |

ಈ ರೀತಿ ಮೇಲ್ಕಂಡ ಬ್ಯಾಕ್ ಲಾಗ್ ಅಭ್ಯರ್ಥಿಯು ತಮ್ಮ ನೇಮಕಾತಿ ಹಕ್ಕನ್ನು ಕಳೆದುಕೊಂಡ ಕಾರಣ ಹಾಗೂ ಮೇಲ್ಕಂಡ ಅಭ್ಯರ್ಥಿಯು ಈ ಜಿಲ್ಲೆಯ ಬ್ಯಾಕ್‌ಲಾಗ್ ಹುದ್ದೆಯಲ್ಲಿ ಕೆಲಸಕ್ಕೆ ಹಾಜರಾಗದ ಕಾರಣ ಸದರಿಯವರ ಬದಲಿಗೆ ಕೆಳಕಂಡ ಬ್ಯಾಕ್‌ಲಾಗ್ ಅಭ್ಯರ್ಥಿಯನ್ನು ನೋಂದಣಿ ಮಹಾಪರಿವೀಕ್ಷಕರು ಮತ್ತು ಮುದ್ರಾಂಕಗಳ ಆಯುಕ್ತರು ರವರು ಉಲ್ಲೇಖ (8)ರ ಅವರ ರೀ-ಅಲಾಟ್ ಮೆಂಟ್ ಆದೇಶದಲ್ಲಿ ಈ ಜಿಲ್ಲೆಗೆ ಅಲಾಟ್ ಮಾಡಿ ಈ ಕೆಳಕಂಡ ಬ್ಯಾಕ್‌ಲಾಗ್ ಅಭ್ಯರ್ಥಿಯನ್ನು ಈ ಜಿಲ್ಲೆಯಲ್ಲಿ ದ್ವಿತೀಯ ದರ್ಜೆ ಸಹಾಯಕರೆಂದು ನೇಮಕ ಮಾಡಿಕೊಳ್ಳುವಂತೆ ನಿರ್ದೇಶಿಸಿದ್ದರ ಮೇರೆ ಕೆಳಕಂಡ ಅಭ್ಯರ್ಥಿಯನ್ನು ಸದರಿ ಬ್ಯಾಕ್‌ಲಾಗ್ ಹುದ್ದೆಯಲ್ಲಿ ನೇಮಕ ಮಾಡಿಕೊಳ್ಳುವ ಸಲುವಾಗಿ ಕೆಳಕಂಡಂತೆ ಆದೇಶ ಹೊರಡಿಸಲಾಗಿದೆ.

**ಆದೇಶ ಸಂಖ್ಯೆ:EST:78:2005-06, ದಿನಾಂಕ: 25ನೇ ಆಗಸ್ಟ್ 2005**

ಪ್ರಸ್ತಾವನೆಯಲ್ಲಿ ವಿವರಿಸಿರುವ ಕಾರಣಗಳ ಹಿನ್ನೆಲೆಯಲ್ಲಿ ಹಾಗೂ ಉಲ್ಲೇಖ (2)ರ ಬ್ಯಾಕ್‌ಲಾಗ್ ನಿಯಮಗಳನ್ವಯ ಪ್ರದತ್ತವಾದ ಅಧಿಕಾರದ ಮೇರೆಗೆ ಉಲ್ಲೇಖ (8) ರಲ್ಲಿನ ಅಲಾಟ್‌ಮೆಂಟ್ ಆದೇಶದಲ್ಲಿ ಕಂಡು ಬಂದ ಕೆಳಕಂಡ ಅಭ್ಯರ್ಥಿಯನ್ನು ಈ ತಕ್ಷಣದಿಂದ ಜಾರಿಗೆ ಬರುವಂತೆ ಮತ್ತು ಮುಂದಿನ ಆದೇಶದವರೆಗೆ ಕೆಳಕಂಡ ಷರತ್ತುಗಳಿಗೆ ಒಳಪಡಿಸಿ ರೂ. 3000-75-3450-100-4450-125-5450 ರವೇತನ ಶ್ರೇಣಿಯಲ್ಲಿ ಇತರೆ ಭತ್ಯೆಗಳು ಸೇರಿದಂತೆ ತಾತ್ಕಾಲಿಕವಾಗಿ ದ್ವಿತೀಯ ದರ್ಜೆ ಸಹಾಯಕರೆಂದು ನೇಮಕ ಮಾಡಲಾಗಿದೆ. ಹಾಗೂ ಸದರಿ ಅಭ್ಯರ್ಥಿಯನ್ನು ಅವರ ಹೆಸರಿನ ಮುಂದೆ ಸೂಚಿಸಿರುವ ಕಛೇರಿಗೆ ದ್ವಿತೀಯ ದರ್ಜೆ ಸಹಾಯಕರೆಂದು ಸ್ಥಳ ನಿಯುಕ್ತಿಗೊಳಿಸಿದೆ.

| ಕ್ರ. ಸಂ. | ಅಭ್ಯರ್ಥಿಯ ಹೆಸರು ಮತ್ತು ವಿಳಾಸ | SC/ST | ಜನ್ಮ ದಿನಾಂಕ | 7.9.2002ರ ದಿನಾಂಕಕ್ಕೆ ಅಭ್ಯರ್ಥಿಯ ವಯಸ್ಸು ವ- ತಿಂ- ದಿ | ವಿದ್ಯಾರ್ಹತೆ ಮತ್ತು ಶೇಕಡಾವಾರು ಅಂಕಗಳು | ಅಭ್ಯರ್ಥಿಯನ್ನು ದ್ವಿತೀಯ ದರ್ಜೆ ಸಹಾಯಕರೆಂದು ನೇಮಕ ಮಾಡಿ ಸ್ಥಳ ನಿಯುಕ್ತಿಗೊಳಿಸಿದ ಕಛೇರಿ ಹೆಸರು | ಯಾವ ಮೀಸಲಾತಿ ಅಡಿಯಲ್ಲಿ ಮತ್ತು ಯಾವ ವರ್ಗೀಕರಣದ ಅಡಿಯಲ್ಲಿ ನೇಮಕ ಮಾಡಲಾಗಿದೆಯೋ ಅದರ ವಿವರ |
|---|---|---|---|---|---|---|---|
| 1. | ಹೇಮಂತ ಕುಮಾರ ಮೇಲಿನಮನಿ S/o ಕೃಷ್ಣಪ್ಪ ರಂಗಪ್ಪ ಮೇಲಿನಮನಿ ಮಹಂತೇಶನಗರ ಪ್ಲಾಟ್ ನಂ.2, ರಾಮದುರ್ಗ-591 123 ಜಿಲ್ಲೆ ಬೆಳಗಾವಿ | SC | 1.6.1973 | 29.03.06 | 71.667 | ಉಪನೋಂದಣಿ ಕಚೇರಿ, ನುಗ್ಗೇಹಳ್ಳಿ ಹಾಸನ ಜಿಲ್ಲೆ | ಪರಿಶಿಷ್ಟ ಜಾತಿ ಗ್ರಾಮೀಣಾ ಅಭ್ಯರ್ಥಿ ಹೆಚ್ಚುವರಿ ಪಟ್ಟಿ |

S.S.L.C. ಅಂಕಪಟ್ಟಿಯ ನೋಂದಣಿ ಸಂಖ್ಯೆ: 216779/April 1990 (ವರ್ಷ) ದ ಪ್ರಕಾರ ಸದರಿ ಅಭ್ಯರ್ಥಿಯ ಜನ್ಮ ದಿನಾಂಕವು 1.6.1973 ಆಗಿರುತ್ತದೆ.

ಈ ನೇಮಕಾತಿ ಆದೇಶವು ಕೆಳಕಂಡ ಷರತ್ತುಗಳಿಗೆ ಒಳಪಟ್ಟಿರುತ್ತದೆ. ಮತ್ತು ಅಭ್ಯರ್ಥಿಗಳು ಈ ಷರತ್ತುಗಳಿಗೆ ಬದ್ಧರಾಗಿರತಕ್ಕದ್ದು.

**ಷರತ್ತುಗಳು:**

1. ಈ ನೇಮಕಾತಿಯು ತಾತ್ಕಾಲಿಕವಾಗಿದ್ದು ಸದರಿ ಅಭ್ಯರ್ಥಿಯನ್ನು ಯಾವುದೇ ನೋಟೀಸ್ ಅಥವಾ ಕಾರಣ ನೀಡದೇ ಯಾವುದೇ ಘಳಿಗೆಯಲ್ಲಾದರೂ ಕೆಲಸದಿಂದ ತೆಗೆದು ಹಾಕುವ ಷರತ್ತಿಗೆ ಒಳಪಟ್ಟು ನೇಮಕಾತಿ ಮಾಡಲಾಗಿದೆ.
2. ಸದರಿ ಅಭ್ಯರ್ಥಿಯನ್ನು ಕರ್ನಾಟಕ ನಾಗರೀಕ ಸೇವಾ (ಸಾಮಾನ್ಯ ನೇಮಕಾತಿ) ನಿಯಮಗಳು 1977 ರಲ್ಲಿನ ನಿಬಂಧನೆಗಳಿಗೆ ಒಳಪಡಿಸಿ ಮತ್ತು ಕರ್ತವ್ಯಕ್ಕೆ ಹಾಜರಾದ ದಿನಾಂಕದಿಂದ ಎರಡು ವರ್ಷದ ಅರ್ಹತಾ ಪರೀಕ್ಷಾ ಅವಧಿಗೆ ಒಳಪಡಿಸಿ ತಾತ್ಕಾಲಿಕವಾಗಿ ನೇಮಕ ಮಾಡಲಾಗಿದೆ.
3. ಈ ನೇಮಕಾತಿಯು ಆಗಿಂದಾಗ್ಗೆ ಜಾರಿಯಲ್ಲಿರುವ ಸೇವಾ ಷರತ್ತುಗಳು, ನಿಯಮ ಮತ್ತು ಆದೇಶಗಳಿಗೆ ಒಳಪಡುತ್ತದೆ. ಹಾಗೂ ಸದರಿ ಅಭ್ಯರ್ಥಿಗಳು ಕೆ.ಸಿ.ಎಸ್.ಆರ್. ಮತ್ತು ಕೆ.ಸಿ.ಎಸ್. (ನಡತೆ) ನಿಯಮಗಳು 1966 ರಲ್ಲಿನ ಮತ್ತು ಕೆ.ಸಿ.ಎಸ್. (ಸಿ.ಸಿ.ಎ) ನಿಯಮಗಳು 1957 ರಲ್ಲಿನ ಹಾಗೂ ಆಗಿಂದಾಗ್ಗೆ ಜಾರಿಗೆ ಬರುವ ಹಾಗೂ ಜಾರಿಯಲ್ಲಿರುವ ಇತರೆ ಸೇವಾ ಷರತ್ತುಗಳಿಗೆ ಮತ್ತು ನಿಬಂಧನೆಗಳಿಗೆ ಒಳಪಡುತ್ತಾರೆ.
4. ಈ ಆದೇಶ ಮುಟ್ಟಿದ 15 (ಹದಿನೈದು) ದಿನಗಳ ಅವಧಿಯೊಳಗೆ ಅಭ್ಯರ್ಥಿಯು ಕೆಲಸಕ್ಕೆ ಹಾಜರಾಗತಕ್ಕದ್ದು. ಒಂದು ವೇಳೆ ನಿಗದಿತ ಅವಧಿಯೊಳಗೆ ಕೆಲಸಕ್ಕೆ ಹಾಜರಾಗದಿದ್ದಲ್ಲಿ ಈ ನೇಮಕಾತಿ ರದ್ದಾಗುವುದು ಹಾಗೂ ನೇಮಕಾತಿ ಬಗ್ಗೆ ಅಭ್ಯರ್ಥಿಯು ಯಾವ ಹಕ್ಕನ್ನೂ ಹೊಂದಿರುವುದಿಲ್ಲವೆಂದು ತಿಳಿಯತಕ್ಕದ್ದು.
5. ಅರ್ಹತಾ ಪರೀಕ್ಷಾ ಅವಧಿಯು ಎರಡು ವರ್ಷಗಳೆಂದು ನಿಗದಿಪಡಿಸಿದೆ. ಈ ಅವಧಿಯೊಳಗೆ 1974ರ ಕರ್ನಾಟಕ ನಾಗರೀಕ ಸೇವಾ (ಸೇವಾ ಮತ್ತು ಕನ್ನಡ ಭಾಷಾ ಪರೀಕ್ಷೆಗಳು) ನಿಯಮಾವಳಿಯಲ್ಲಿ ಈ ಇಲಾಖೆಯ ದ್ವಿತೀಯ ದರ್ಜೆ ಸಹಾಯಕರ ಹುದ್ದೆಗಳಿಗೆ ನಿಗದಿಪಡಿಸಿದ ಇಲಾಖಾ ಪರೀಕ್ಷೆಗಳಲ್ಲಿ ಅಭ್ಯರ್ಥಿಯು ಕಡ್ಡಾಯವಾಗಿ ತೇರ್ಗಡೆ ಹೊಂದತಕ್ಕದ್ದು. ಇದಕ್ಕೆ ತಪ್ಪಿದಲ್ಲಿ ಕೆ.ಸಿ.ಎಸ್. (ಪ್ರೊಬೇಷನ್) ರೂಲ್ಸ್ 1977ರ ಅಡಿಯಲ್ಲಿ ಕಟ್ಟುನಿಟ್ಟಿನ ಕ್ರಮ ಜರುಗಿಸಲಾಗುವುದು.
6. ಅಭ್ಯರ್ಥಿಯು ತಮಗೆ ವಹಿಸಿದ ಕೆಲಸ ಕಾರ್ಯಗಳನ್ನು ತೃಪ್ತಿಕರವಾಗಿ ಮಾಡತಕ್ಕದ್ದು.
7. ವಿದ್ಯಾರ್ಹತೆಯ ಬಗ್ಗೆ ಇರುವ ಮೂಲ ಪ್ರಮಾಣ ಪತ್ರಗಳನ್ನು ಹಾಜರಾಗುವ ಕಛೇರಿಯಲ್ಲಿ ಆ ಕಛೇರಿಯ ಮುಖ್ಯಸ್ಥರ ಮುಂದೆ ಹಾಜರುಪಡಿಸತಕ್ಕದ್ದು.
8. ಜನ್ಮ ದಿನಾಂಕದ ಬಗ್ಗೆ ಮೂಲ ಪ್ರಮಾಣ ಪತ್ರವನ್ನು ಹಾಜರಾಗುವ ಕಛೇರಿಯಲ್ಲಿ ಆ ಕಛೇರಿಯ ಮುಖ್ಯಸ್ಥರ ಮುಂದೆ ಹಾಜರುಪಡಿಸತಕ್ಕದ್ದು.
9. ಭಾರತದ ಸಂವಿಧಾನಕ್ಕೆ ಬದ್ಧರಾಗಿರುವ ಬಗ್ಗೆ ನಿಷ್ಠೆ ಪ್ರಮಾಣ ಪತ್ರವನ್ನು (ಪ್ರತಿಜ್ಞಾ ವಿಧಿ) ಬರೆದುಕೊಡತಕ್ಕದ್ದು.
10. ಕೆಲಸಕ್ಕೆ ಹಾಜರಾಗುವ ಮುನ್ನ ಅಭ್ಯರ್ಥಿಯು ಸಂಬಂಧಪಟ್ಟ ಜಿಲ್ಲಾ ಸರ್ಜನ್‌ನಿಂದ ದೈಹಿಕ ಪ್ರಮಾಣ ಪತ್ರವನ್ನು ನಿಗದಿತ ನಮೂನೆಯಲ್ಲಿ ಪಡೆದು ಹಾಜರಾಗುವ ಕಛೇರಿಯಲ್ಲಿ ಆ ಕಛೇರಿಯ ಮುಖ್ಯಸ್ಥರ ಮುಂದೆ ಹಾಜರುಪಡಿಸತಕ್ಕದ್ದು.
11. ಅಭ್ಯರ್ಥಿಯು ಕಡೆಯದಾಗಿ ಹಾಜರಾಗಿದ್ದ ಶಾಲೆಯ ಮುಖ್ಯೋಪಾಧ್ಯಾಯರು ನೀಡಿರುವ ನಡತೆ ಪ್ರಮಾಣ ಪತ್ರವನ್ನು ಹಾಜರಾಗುವ ಕಛೇರಿಯಲ್ಲಿ ಆ ಕಛೇರಿಯ ಮುಖ್ಯಸ್ಥರ ಮುಂದೆ ಹಾಜರುಪಡಿಸತಕ್ಕದ್ದು.
12. ಅಭ್ಯರ್ಥಿಯು ಮದುವೆಯಾಗಿದ್ದಲ್ಲಿ ಒಬ್ಬರೇ ಪತಿ ಅಥವಾ ಪತ್ನಿ ಹೊಂದಿರುವ ಬಗ್ಗೆ ಕೆ.ಸಿ.ಎಸ್. (ನಡತೆ) ನಿಯಮಗಳು 1966 ರಲ್ಲಿನ ನಿಯಮ 28 ರೀತ್ಯಾ ಹಾಜರಾಗುವ ಕಛೇರಿಯಲ್ಲಿ ಆ ಕಛೇರಿಯ ಮುಖ್ಯಸ್ಥರ ಮುಂದೆ ಘೋಷಣೆ ಹಾಜರ್‌ಪಡಿಸತಕ್ಕದ್ದು.
13. ಅಭ್ಯರ್ಥಿಯು ತಮ್ಮ ಜಾತಿ, ಜನ್ಮ ದಿನಾಂಕ, ವಿದ್ಯಾರ್ಹತೆ ಇತ್ಯಾದಿಯಾಗಿ ಯಾವುದೇ ವಿಚಾರದಲ್ಲಿ ಅಭ್ಯರ್ಥಿಯು ನೀಡಿರುವ ವಿವರಗಳು ಸುಳ್ಳೆಂದಾಗಲೀ ಅಥವಾ ತಪ್ಪೆಂದಾಗಲೀ ತಿಳಿದು ಬಂದಲ್ಲಿ ಅಂತಹ ಅಭ್ಯರ್ಥಿಯ ವಿರುದ್ಧ ಭಾರತೀಯ ದಂಡ ಸಂಹಿತೆಯಲ್ಲಿನ ಸೂಕ್ತ ಕಲಂಗಳ ಅಡಿಯಲ್ಲಿ ಕ್ರಮ ಕೈಗೊಳ್ಳಲಾಗುವುದು. ಹಾಗೂ ಕೆ.ಸಿ.ಎಸ್ (ಸಿ.ಸಿ.ಎ) ನಿಯಮಗಳು 1957ರ ಅಡಿಯಲ್ಲಿ ಶಿಸ್ತು ಕ್ರಮ ಕೈಗೊಳ್ಳಲಾಗುವುದು.
14. ಮಹಿಳಾ ಮೀಸಲಾತಿ ಅಡಿಯಲ್ಲಿ ಆಯ್ಕೆಯಾದ ಎಲ್ಲಾ ಮಹಿಳಾ ಅಭ್ಯರ್ಥಿಗಳು ಗೌರವಾನ್ವಿತ ಭಾರತದ ಸರ್ವೋಚ್ಚ ನ್ಯಾಯಾಲಯದಲ್ಲಿ ದಾಖಲಾಗಿರುವ ರಿಟ್ ಅರ್ಜಿ (ಸಿವಿಲ್) ಸಂಖ್ಯೆ 232/99 (ಶ್ರೀ ಬಿ.ಎಲ್. ನಾರಾಯಣ - vs - ಕರ್ನಾಟಕ ರಾಜ್ಯ ಮತ್ತು ಇತರರು) ಇದರಲ್ಲಿ ಆಗುವ ಅಂತಿಮ ತೀರ್ಪಿಗೆ ಬದ್ಧರಾಗಿರತಕ್ಕದ್ದು ಹಾಗೂ ದ್ವಿತೀಯ ದರ್ಜೆ ಸಹಾಯಕರ ಹುದ್ದೆಯ ಮೇಲೆ ಯಾವುದೇ ಹಕ್ಕನ್ನು ಹೊಂದಿರತಕ್ಕದಲ್ಲ ಅಥವಾ ಯಾವುದೇ ಹಕ್ಕನ್ನು ಸಾಧಿಸತಕ್ಕದ್ದಲ್ಲವೆಂದು ತಿಳಿಯತಕ್ಕದ್ದು ಹಾಗೂ ಸದರಿ ರಿಟ್ ಅರ್ಜಿ (ಸಿವಿಲ್) ಸಂಖ್ಯೆ: 232/99 ರಲ್ಲಿ ಆಗುವ ಅಂತಿಮ ತೀರ್ಪಿಗೆ ಬದ್ಧಳಾಗಿರುತ್ತೇನೆ ಎಂಬ ಬಗ್ಗೆ 20/- ರೂ. ಗಳ ಛಾಪಾ ಕಾಗದದಲ್ಲಿ ಮುಚ್ಚಳಿಕೆ ನಮೂನೆ-3 ಅನ್ನು ಈ ಕಛೇರಿಗೆ ಬರೆದುಕೊಡತಕ್ಕದ್ದು.
15. ಅಭ್ಯರ್ಥಿಗಳು ಸಲ್ಲಿಸಿರುವ ಅಂಕಪಟ್ಟಿಗಳು ಮತ್ತು ಮೀಸಲಾತಿ ಪ್ರಮಾಣ ಪತ್ರಗಳು ಹಾಗೂ ಜಾತಿ ಪ್ರಮಾಣ ಪತ್ರಗಳು ಸಕ್ಷಮ ಪ್ರಾಧಿಕಾರದಿಂದ ಸತ್ಯಾಪನೆಗೆ ಒಳಪಡುತ್ತವೆ.
16. ಒಂದು ವೇಳೆ ಅಭ್ಯರ್ಥಿಯು ಸಲ್ಲಿಸಿರುವ ಅಂಕಪಟ್ಟಿಗಳು ಮತ್ತು ಮೀಸಲಾತಿ ಪ್ರಮಾಣ ಪತ್ರಗಳು ಹಾಗೂ ಜಾತಿ ಪ್ರಮಾಣ ಪತ್ರಗಳು ಸುಳ್ಳು ಅಥವಾ ನಕಲಿ ಎಂದು ದೃಢಪಟ್ಟಲ್ಲಿ ಅಂತಹ ಅಭ್ಯರ್ಥಿಗಳ ಆಯ್ಕೆಯನ್ನು ಮತ್ತು ನೇಮಕಾತಿಯನ್ನು ಶಾಶ್ವತವಾಗಿ ರದ್ದುಪಡಿಸಲಾಗುವುದು ಹಾಗೂ ಅಭ್ಯರ್ಥಿಯ ವಿರುದ್ಧ ಭಾರತೀಯ ದಂಡ ಸಂಹಿತೆಯಲ್ಲಿನ ಸೂಕ್ತ ಕಲಂಗಳ ಅಡಿಯಲ್ಲಿ ಕ್ರಮ ಕೈಗೊಳ್ಳಲಾಗುವುದು ಹಾಗೂ KCS (CCA) ನಿಯಮಗಳು 1957ರ ಅಡಿಯಲ್ಲಿ ಶಿಸ್ತು ಕ್ರಮ ಕೈಗೊಳ್ಳಲಾಗುವುದು. ಇದಕ್ಕೆ ಬದ್ಧನಾಗಿರುತ್ತೇನೆ ಎಂಬ ಬಗ್ಗೆ ಅಭ್ಯರ್ಥಿಯು 20.00 ರೂಗಳ ಛಾಪಾ ಕಾಗದದಲ್ಲಿ ಮುಚ್ಚಳಿಕೆ ನಮೂನೆ-1 ಅನ್ನು ಈ ಕಛೇರಿಗೆ ಬರೆದುಕೊಡತಕ್ಕದ್ದು.
17. ಅಭ್ಯರ್ಥಿಗಳು ಪರಿಶಿಷ್ಟ ಜಾತಿ ಮತ್ತು ಪರಿಶಿಷ್ಟ ಪಂಗಡದ ಅಭ್ಯರ್ಥಿಗಳಲ್ಲವೆಂದು ಸತ್ಯಾಪನೆಯಿಂದ ದೃಢಪಟ್ಟಲ್ಲಿ ಅಂತಹ ಅಭ್ಯರ್ಥಿಗಳ ನೇಮಕಾತಿಯನ್ನು ಶಾಶ್ವತವಾಗಿ ಯಾವುದೇ ಸೂಚನೆ ಇಲ್ಲದೇ ರದ್ದುಪಡಿಸಲಾಗುವುದು.

18. ಗ್ರಾಮೀಣ ಮೀಸಲಾತಿ ಅಡಿಯಲ್ಲಿ ಆಯ್ಕೆಗೊಂಡ ಅಭ್ಯರ್ಥಿಗಳು ಗ್ರಾಮೀಣ ಅಭ್ಯರ್ಥಿಗಳಲ್ಲವೆಂದು ಹಾಗೂ ಮಾಜಿ ಸೈನಿಕರ ಮೀಸಲಾತಿಯಲ್ಲಿ ಆಯ್ಕೆಗೊಂಡವರು ಮಾಜಿ ಸೈನಿಕರಲ್ಲವೆಂದು ದೃಢಪಟ್ಟಲ್ಲಿ ಅಂತಹ ಅಭ್ಯರ್ಥಿಗಳ ನೇಮಕಾತಿಯನ್ನು ಶಾಶ್ವತವಾಗಿ ಯಾವುದೇ ಸೂಚನೆ ಇಲ್ಲದೇ ರದ್ದುಪಡಿಸಲಾಗುವುದು.
19. ಇದೇ ರೀತಿ ಯೋಜನಾ ನಿರಾಶ್ರಿತರ ಮೀಸಲಾತಿ ಅಡಿಯಲ್ಲಿ ಆಯ್ಕೆಗೊಂಡವರು ಯೋಜನಾ ನಿರಾಶ್ರಿತ ಅಭ್ಯರ್ಥಿಗಳಲ್ಲವೆಂದು ಮತ್ತು ಅಂಗವಿಕಲರ ಮೀಸಲಾತಿ ಅಡಿಯಲ್ಲಿ ಆಯ್ಕೆಗೊಂಡವರು ಅಂಗವಿಕಲ ಅಭ್ಯರ್ಥಿಗಳಲ್ಲವೆಂದು ದೃಢಪಟ್ಟಲ್ಲಿ ಅಂತಹ ಅಭ್ಯರ್ಥಿಗಳ ನೇಮಕಾತಿಯನ್ನು ಶಾಶ್ವತವಾಗಿ ಯಾವುದೇ ಸೂಚನೆ ಇಲ್ಲದೇ ರದ್ದುಪಡಿಸಲಾಗುವುದು.
20. ಈ ನೇಮಕಾತಿ ಆದೇಶವು ಯಾವುದೇ ಸಂದರ್ಭದಲ್ಲಾದರೂ ತಿದ್ದೋಲೆ ಮತ್ತು ಮಾರ್ಪಾಡಿಗೆ ಒಳಪಟ್ಟಿರುತ್ತದೆ.
21. ನೇಮಕಾತಿ ಮಾಡಿರುವ ಸ್ಥಳದ ಅಥವಾ ಕಛೇರಿಯ ಮಾರ್ಪಾಡಿಗಾಗಿ ಯಾವುದೇ ಮನವಿಗಳನ್ನು ಯಾವುದೇ ಕಾರಣಕ್ಕಾಗಲೀ ಪುರಸ್ಕರಿಸಲಾಗುವುದಿಲ್ಲ.
22. ಅಭ್ಯರ್ಥಿಯು KGID ಯಲ್ಲಿ ಸರ್ಕಾರಿ ವಿಮೆಯನ್ನು ಕಡ್ಡಾಯವಾಗಿ ಮಾಡತಕ್ಕದ್ದು.
23. ಈ ನೇಮಕಾತಿಗಾಗಿ ಅರ್ಜಿ ಸಲ್ಲಿಸಿರುವ ಅಭ್ಯರ್ಥಿಗಳ ಪೈಕಿ ಬೇರೆ ಇನ್ನಾವುದೇ ಅಭ್ಯರ್ಥಿಯು ಅವರ ಆಯ್ಕೆಯನ್ನು ದಾಖಲೆ ಸಹಿತ establish ಮಾಡಿದಲ್ಲಿ ಅಥವಾ ನನ್ನ ನೇಮಕಾತಿಯು ಅಸಿಂಧುವೆಂದು ದಾಖಲೆಗಳ ಸಹಿತ ಸಾಬೀತುಪಡಿಸಿದಲ್ಲಿ ನನ್ನ ನೇಮಕಾತಿಯನ್ನು ಯಾವುದೇ ಸೂಚನೆ ಇಲ್ಲದೇ ಶಾಶ್ವತವಾಗಿ ರದ್ದುಗೊಳಿಸಿ ನನ್ನ ಬದಲಿಗೆ ಬೇರೊಬ್ಬರನ್ನು ಆಯ್ಕೆ ಮಾಡಬಹುದು ಎಂಬ ಬಗ್ಗೆ ಅಭ್ಯರ್ಥಿಯು 20/- ರೂ ಛಾಪಾ ಕಾಗದದಲ್ಲಿ ಮುಚ್ಚಳಿಕೆ ನಮೂನೆ-2 ಅನ್ನು ಈ ಕಛೇರಿಗೆ ಬರೆದುಕೊಡತಕ್ಕದ್ದು.
24. ಎರಡು ವರ್ಷದ ಪರೀಕ್ಷಾರ್ಥ ಅವಧಿಯಲ್ಲಿ ಅಭ್ಯರ್ಥಿಗಳು ತಮ್ಮ ವರ್ಗಾವಣೆಗಾಗಿ ರಾಜಕೀಯ ಅಥವಾ ಇನ್ನಾವುದೇ ರೀತಿಯ ಒತ್ತಡ ತಂದಲ್ಲಿ ಅಂತಹವರ ವಿರುದ್ಧ ಕಾನೂನು ರೀತ್ಯಾ ಶಿಸ್ತು ಕ್ರಮ ಜರುಗಿಸಲಾಗುವುದು.

ಪಿ.ಆರ್. 1243 ನೇಮಕಾತಿ ಪ್ರಾಧಿಕಾರಿ ಹಾಗೂ ಜಿಲ್ಲಾ ನೋಂದಣಾಧಿಕಾರಿಗಳು, ಹಾಸನ ಜಿಲ್ಲೆ, ಹಾಸನ.

## ಜಿಲ್ಲಾ ಸಮಾಜ ಕಲ್ಯಾಣಾಧಿಕಾರಿಗಳ ಕಛೇರಿ, ಚಿಕ್ಕಮಗಳೂರು,

**ಪ್ರಕಟಣೆ ಸಂ:ಜಿಸಕಅ:ಎಸ್‌ಡಬ್ಲ್ಯೂ-7:ಸಿಆರ್-7:2005-06, ದಿನಾಂಕ: 26ನೇ ಆಗಸ್ಟ್ 2005**

**ವಿಷಯ:** ಪ.ಜಾತಿಗೆ ಸೇರಿದ ಕಾನೂನು ಪದವೀಧರರಿಗೆ ನ್ಯಾಯಾಂಗ ಆಡಳಿತದಲ್ಲಿ ತರಬೇತಿ ನೀಡುವ ಕುರಿತು.

**ಉಲ್ಲೇಖ:** ಸರ್ಕಾರದ ಆದೇಶ ಸಂ:ಎಸ್‌ಡಬ್ಲ್ಯೂಎಲ್-68:ಎಸ್‌ಡಬ್ಲ್ಯೂಎ:89:ದಿನಾಂಕ:2.11.1990.

ಚಿಕ್ಕಮಗಳೂರು ಜಿಲ್ಲೆಯಲ್ಲಿರುವ ಪ.ಜಾತಿಗೆ ಸೇರಿದ ಕಾನೂನು ಪದವೀಧರರಿಗೆ 2005-06ನೇ ಸಾಲಿಗೆ ಆಡಳಿತ ನ್ಯಾಯಾಧೀಕರಣದಲ್ಲಿ ನಾಲ್ಕು ವರ್ಷದ ತರಬೇತಿಯನ್ನು ನೀಡುವ ಸಲುವಾಗಿ ಅರ್ಹ ವಿದ್ಯಾರ್ಥಿಗಳಿಂದ ನಿಗದಿತ ನಮೂನೆಯಲ್ಲಿ ಅರ್ಜಿಯನ್ನು ಕರೆಯಲಾಗಿದೆ. ಈ ತರಬೇತಿಯನ್ನು ಪಡೆಯಲು ಇಚ್ಛಿಸುವ ಅಭ್ಯರ್ಥಿಗಳು ಈ ಕೆಳಕಂಡ ಅರ್ಹತೆಯನ್ನು ಹೊಂದಿರಬೇಕು.

1. ಅಭ್ಯರ್ಥಿಗಳು ಪರಿಶಿಷ್ಟ ಜಾತಿಗೆ ಸೇರಿದವರಾಗಿರಬೇಕು.
2. ಈ ಅಭ್ಯರ್ಥಿಗಳು ಆಡಳಿತ ನ್ಯಾಯಾಧೀಕರಣದಲ್ಲಿ ವೃತ್ತಿಯನ್ನು ಕೈಗೊಳ್ಳಲು ಅರ್ಹತೆ ಹೊಂದುವ ಕಾನೂನು ಪದವಿಯನ್ನು ಪಡೆದಿರಬೇಕು.
3. ಜಿಲ್ಲಾ ಮಟ್ಟದ ಆಯ್ಕೆ ಸಮಿತಿಯ ಮೂಲಕ ಅಭ್ಯರ್ಥಿಯನ್ನು ಸಂದರ್ಶನಕ್ಕೆ ಕರೆದು ಆಯ್ಕೆ ಮಾಡಲಾಗುವುದು ಹಾಗೂ ಅವರನ್ನು ನಾಲ್ಕು ವರ್ಷದ ತರಬೇತಿಗೆ ಸರ್ಕಾರಿ ಅಭಿಯೋಜಕರ ಬಳಿ ತರಬೇತಿಗೆ ನಿಯೋಜಿಸಲಾಗುವುದು.
4. ಈ ತರಬೇತಿಯ ಅವಧಿಯಲ್ಲಿ ಹಾಜರಾತಿ ಹಾಗೂ ದಿನಚರಿಯನ್ನು ಪಡೆದು ಅದನ್ನು ಪರಿಶೀಲಿಸಿ ಪ್ರತಿ ತಿಂಗಳು ರೂ. 1,000.00 (ಒಂದು ಸಾವಿರ) ತರಬೇತಿ ಭತ್ಯೆಯನ್ನು ಹಾಜರಾತಿ ಅನುಸರಿಸಿ ಪಾವತಿಸಲಾಗುವುದು.
5. ಅಭ್ಯರ್ಥಿಗಳು ಸರ್ಕಾರದಿಂದ ರೂಪಿಸಲಾದ ನಿಯಮಗಳಿಗೆ ಬದ್ಧರಾಗಿರುವ ಬಗ್ಗೆ ತರಬೇತಿಯನ್ನು ಮಧ್ಯದಲ್ಲೆ ಬಿಡದಿರುವ ಬಗ್ಗೆ ಒಂದು ಮುಚ್ಚಳಿಕೆ ಪತ್ರವನ್ನು 15 ರೂ.ಗಳ ಛಾಪಾ ಕಾಗದದ ಮೇಲೆ ಬರೆದು ಕೊಡಬೇಕು.
6. ತರಬೇತಿಗೆ ಅರ್ಜಿಯನ್ನು ಸಲ್ಲಿಸಲು ಇಚ್ಛಿಸುವ ಅಭ್ಯರ್ಥಿಗಳು ದ್ವಿಪ್ರತಿಯಲ್ಲಿ ಕೊನೆಯ ದಿನಾಂಕದೊಳಗೆ ಭರ್ತಿ ಮಾಡಿ ಎಸ್.ಎಸ್.ಎಲ್.ಸಿ. ಗೆ ಮೇಲ್ಪಟ್ಟ ಎಲ್ಲಾ ಪರೀಕ್ಷೆಗಳ ಅಂಕಪಟ್ಟಿ, ಜಾತಿ ದೃಢೀಕರಣ ಪತ್ರಗಳನ್ನು ಸಕ್ಷಮ ಅಧಿಕಾರಿಗಳಿಂದ ಪಡೆದು ನ್ಯಾಯವಾದಿ ವೃತ್ತಿಯನ್ನು ಪ್ರಾರಂಭಿಸಲು ಬೇಕಾಗುವ ಬಾರ್ ಕೌನ್ಸಿಲರ್ ನೋಂದಣಿ ಪ್ರಮಾಣ ಪತ್ರದ ಪ್ರತಿಯೊಂದಿಗೆ ಅರ್ಜಿ ಸಲ್ಲಿಸಬೇಕು.
7. ಅರ್ಜಿ ಸಲ್ಲಿಸುವ ದಿನಾಂಕಕ್ಕೆ 2 ವರ್ಷಗಳ ಒಳಗೆ ಕಾನೂನು ಪದವಿಯನ್ನು ಪಡೆದ ಪ.ಜಾತಿ ವಿದ್ಯಾರ್ಥಿಗಳು ಮಾತ್ರ ಅರ್ಹರಾಗಿರುತ್ತಾರೆ.
8. ಅರ್ಜಿ ಸ್ವೀಕರಿಸುವ ಕೊನೆಯ ದಿನಾಂಕ ಅಭ್ಯರ್ಥಿಗಳ ವಯಸ್ಸು 35 ವರ್ಷವನ್ನು ಮೀರಿರಬಾರದು.
9. ಆಯ್ಕೆಯಾದ ಅಭ್ಯರ್ಥಿಯು ಯಾವುದೇ ನೌಕರಿಯಲ್ಲಿರಬಾರದು ಅಥವಾ ತರಬೇತಿ ಸರ್ಕಾರಿ ಖಾಸಗಿ ಸೇವೆಗಳಲ್ಲಿ ಸೇರಿರಬಾರದು.
10. ಪೂರ್ತಿಯಾಗಿ ಭರ್ತಿ ಮಾಡಿದ ಅರ್ಜಿಗಳನ್ನು ಕಾರ್ಯದರ್ಶಿ, ಜಿಲ್ಲಾ ಮಟ್ಟದ ಆಯ್ಕೆ ಸಮಿತಿ, ಜಿಲ್ಲಾ ಸಮಾಜ ಕಲ್ಯಾಣಾಧಿಕಾರಿಗಳು, ಚಿಕ್ಕಮಗಳೂರು ಇವರಿಗೆ ದಿನಾಂಕ 12.9.2005ರ ಸಂಜೆ 5.00 ಗಂಟೆಯೊಳಗಾಗಿ ತಲುಪಿಸಬೇಕು.
11. ನಿಗದಿತ ನಮೂನೆಯ ಅರ್ಜಿ ಫಾರಂಗಳನ್ನು ಈ ಕಛೇರಿಯ ವೇಳೆಯಲ್ಲಿ ಉಚಿತವಾಗಿ ಪಡೆದುಕೊಳ್ಳಬಹುದು.

ಪಿ.ಆರ್. 1244 ಜಿಲ್ಲಾ ಸಮಾಜ ಕಲ್ಯಾಣಾಧಿಕಾರಿ, ಚಿಕ್ಕಮಗಳೂರು.

## ಕಾರ್ಮಿಕ ಅಧಿಕಾರಿ ಹಾಗೂ ಕಾರ್ಮಿಕ ನಷ್ಟ ಪರಿಹಾರ ಆಯುಕ್ತರ ನ್ಯಾಯಾಲಯ, ಉಪವಿಭಾಗ-1 ಚಿಕ್ಕಮಗಳೂರು ಜಿಲ್ಲೆ

**ಸಂಖ್ಯೆ: ಕಾಪಕಾ:ಎಫ್:08:2003**

**ಅರ್ಜಿದಾರರು** ವಿರುದ್ಧ **ಪ್ರತಿವಾದಿಗಳು**

ಮಂಜುನಾಥ್ ಬಿನ್ ಲೇಟ್ ಪೊನ್ನುಸ್ವಾಮಿ
ಹಾಗೂ 3 ಜನರು ಹೊಸಳ್ಳಿ ವಾಸಿಗಳು ಆಲ್ದೂರು
ಅಂಚೆ, ಚಿಕ್ಕಮಗಳೂರು ತಾಲ್ಲೂಕು.

1. ಮಾಲೀಕರು, ಬೆಳಗೋಡು ಕಾಫಿ ಎಸ್ಟೇಟ್, ಆಲ್ದೂರು ಅಂಚೆ, ಚಿಕ್ಕಮಗಳೂರು ತಾಲ್ಲೂಕು
2. ಯುನೈಟೆಡ್ ಇಂಡಿಯ ಇನ್ಸೂರೆನ್ಸ್ ಕಂಪೆನಿ, ಚಿಕ್ಕಮಗಳೂರು ಶಾಖೆ, ಚಿಕ್ಕಮಗಳೂರು.

**ಪ್ರಕಟಣೆ**

ಪೊನ್ನುಸ್ವಾಮಿ ಎಂಬುವವರು ಪ್ರತಿವಾದಿಯಲ್ಲಿ ಕೆಲಸದ ಮೇಲಿದ್ದಾಗ ದಿನಾಂಕ:12.3.2003 ರಂದು ಅಪಘಾತ ಉಂಟಾಗಿ ಮೃತಪಟ್ಟಿರುವ ಬಗ್ಗೆ ಪರಿಹಾರ ಕೋರಿ ಮೇಲ್ಕಂಡ ಅರ್ಜಿದಾರರು ಅರ್ಜಿಯನ್ನು ಈ ನ್ಯಾಯಾಲಯದಲ್ಲಿ ಸಲ್ಲಿಸಿರುತ್ತಾರೆ.

ಆದ್ದರಿಂದ ಸಾರ್ವಜನಿಕರಿಗೆ ಮತ್ತು ಸಂಬಂಧಪಟ್ಟವರಿಗೆ ಈ ಮೂಲಕ ತಿಳಿಸುವುದೇನೆಂದರೆ ಈ ಬಗ್ಗೆ ತಮ್ಮ ಆಕ್ಷೇಪಣೆಗಳೇನಾದರೂ ಇದ್ದರೆ ಹಾಗೂ ಅರ್ಜಿದಾರರಲ್ಲದೆ ತಾವೇನಾದರೂ ಮೃತರ ನಿಜವಾದ ಅವಲಂಬಿತರು ಎಂದು ಕೇಳಿಕೊಳ್ಳುವುದಾದರೆ ಅಂತಹವರು ಈ ಪ್ರಕಟಣೆ ಕರ್ನಾಟಕ ರಾಜ್ಯಪತ್ರದಲ್ಲಿ ಪ್ರಕಟವಾದ 30 ದಿನಗಳೊಳಗಾಗಿ ತಮ್ಮ ಆಕ್ಷೇಪಣೆ ಅಥವಾ ಅರ್ಜಿಗಳನ್ನು ಈ ನ್ಯಾಯಾಲಯಕ್ಕೆ ಸಲ್ಲಿಸತಕ್ಕದ್ದು. ನಿಗದಿಪಡಿಸಿದ ಅವಧಿಯಲ್ಲಿ ಯಾರಿಂದಲೂ ಆಕ್ಷೇಪಣೆಗಳಾಗಲೀ ಅಥವಾ ಅರ್ಜಿಗಳಾಗಲೀ ಬಾರದೆ ಇದ್ದಲ್ಲಿ ಅರ್ಜಿದಾರರನ್ನು ಹೊರತುಪಡಿಸಿ ಮೃತನ ಅವಲಂಬಿತರು ಯಾರು ಇಲ್ಲ ಎಂದು ಪರಿಗಣಿಸಿ ಮೇಲ್ಕಂಡ ಅರ್ಜಿದಾರರ ಕ್ಲೇಮ್ ಅರ್ಜಿಯ ಬಗ್ಗೆ ಮುಂದಿನ ಕ್ರಮ ಕೈಗೊಳ್ಳಲಾಗುವುದು.

**ಆರ್.ಬಿ. ಬಾಗೇವಾಡಿ**

ಪಿ.ಆರ್. 1245 ಕಾರ್ಮಿಕ ಅಧಿಕಾರಿ ಹಾಗೂ ಕಾರ್ಮಿಕ ನಷ್ಟ ಪರಿಹಾರ ಆಯುಕ್ತರು,
ಉಪವಿಭಾಗ-1, ಚಿಕ್ಕಮಗಳೂರು.

**ಆರ್ಥಿಕ ಇಲಾಖೆ**

**ಅಧಿಸೂಚನೆ ಸಂಖ್ಯೆ:ಆಇ 308 ರಾಲೆಪ 2005, ಬೆಂಗಳೂರು, ದಿನಾಂಕ: 31ನೇ ಆಗಸ್ಟ್ 2005**

ಶ್ರೀಮತಿ ಸಲ್ಮಾನಾಜ್ಞಿ, ಸಹಾಯಕ ನಿಯಂತ್ರಕರು (ಸ್ವ.ಪ್ರ), ರಾಜ್ಯ ಲೆಕ್ಕ ಪತ್ರ ಇಲಾಖೆ ಓಓಡಿ ಲೆಕ್ಕಾಧಿಕಾರಿ, ಪ್ರಾದೇಶಿಕ ಜಂಟಿ ನಿರ್ದೇಶಕರ ಕಛೇರಿ, ಕಾಲೇಜು ಶಿಕ್ಷಣ ಇಲಾಖೆ, ಶಿವಮೊಗ್ಗ ಇವರಿಗೆ ದಿನಾಂಕ: 31.8.05ರ ಅಪರಾಹ್ನದಿಂದ ಜಾರಿಗೆ ಬರುವಂತೆ ಕರ್ನಾಟಕ ನಾಗರೀಕ ಸೇವಾ ನಿಯಮಾವಳಿಗಳ ನಿಯಮ 285(1)(ಎ) ರನ್ವಯ ಸೇವೆಯಿಂದ ಸ್ವಇಚ್ಛಾ ನಿವೃತ್ತಿ ಹೊಂದಲು ಸರ್ಕಾರವು ಅನುಮತಿ ನೀಡಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 1246 **ಎನ್. ಪ್ರಭಾಕರ್**

ಸರ್ಕಾರದ ಅಧೀನ ಕಾರ್ಯದರ್ಶಿ, ಆರ್ಥಿಕ ಇಲಾಖೆ (ಆಡಳಿತ)

**ಸಹಕಾರ ಸಂಘಗಳ ಸಂಯುಕ್ತ ನಿಬಂಧಕರ ನ್ಯಾಯಾಲಯ, ಬೆಂಗಳೂರು ಪ್ರಾಂತ,**
**ಚಾಮರಾಜಪೇಟೆ, ಬೆಂಗಳೂರು - 560 018**

**ವಿಷಯ:** ಸಮಾಪನೆಗೊಂಡಿರುವ ಜಗಳೂರು ತಾಲ್ಲೂಕು ಕಲ್ಲುಕುಟ್ಟುವವರ ಮತ್ತು ಮಣ್ಣು ಅಗೆಯುವವರ ಸಹಕಾರ ಸಂಘ ನಿಯಮಿತ, ಜಗಳೂರು ಇದರ ನೊಂದಣಿ ಸಂಖ್ಯೆ ರದ್ದುಪಡಿಸುವ ಬಗ್ಗೆ.

**ಉಲ್ಲೇಖ:**
1. ಈ ಕಛೇರಿಯ ಸಮಾಪನೆ ಆದೇಶ ದಿ.9.4.01.
2. ಸಹಕಾರ ಸಂಘಗಳ ಉಪ ನಿಬಂಧಕರು, ದಾವಣಗೆರೆ ರವರ ಪತ್ರ ಸಂಖ್ಯೆ:ಡಿಆರ್/ಡಿವಿಜಿ/ಎಲ್‌ಕ್ಯೂಡಿ/62/91-92, ದಿನಾಂಕ: 30.7.2005.

**ಪ್ರಸ್ತಾವನೆ:**

ಜಗಳೂರು ತಾಲ್ಲೂಕು ಕಲ್ಲು ಕುಟ್ಟುವವರ ಮತ್ತು ಮಣ್ಣು ಅಗೆಯುವವರ ಸಹಕಾರ ಸಂಘ ನಿಯಮಿತ, ಜಗಳೂರು ತಾಲ್ಲೂಕು, ದಾವಣಗೆರೆ, ಈ ಸಹಕಾರ ಸಂಘವು ದಿನಾಂಕ: 25.1.1985 ರಂದು ನೋಂದಣಿಯಾಗಿದ್ದು, ಸಂಘವು ಸ್ಥಗಿತಗೊಂಡಿದ್ದರಿಂದ ಸಹಕಾರ ಸಂಘಗಳ ಉಪ ನಿಬಂಧಕರು, ದಾವಣಗೆರೆಯವರ ಶಿಫಾರಸ್ಸಿನನ್ವಯ ಉಲ್ಲೇಖ (1) ರ ಪತ್ರ ದಿನಾಂಕ: 9.4.2001 ರಂದು ಸದರಿ ಸಂಘವನ್ನು ಸಮಾಪನೆಗೊಳಿಸಿ, ಸಹಕಾರ ಸಂಘಗಳ ನಿರೀಕ್ಷಕರು, ಜಗಳೂರುರವರನ್ನು ಸಮಾಪನಾಧಿಕಾರಿಯಾಗಿ ನೇಮಿಸಲಾಗಿದ್ದು, ಸದರಿಯವರು ಪ್ರಭಾರ ವಹಿಸಿಕೊಂಡು ದಿನಾಂಕ: 1.7.2005 ರಂದು ನಡೆಸಿದ ಸಭೆಯ ನಡವಳಿಕೆಯಲ್ಲಿ ಸಂಘದ ಆಸ್ತಿ-ಜವಾಬ್ದಾರಿಗಳನ್ನು ವಿಲೇಗೊಳಿಸಲು ತೀರ್ಮಾನಿಸಿ, ದಿನಾಂಕ: 1.4.2004 ರಿಂದ 1.7.2005 ರವರೆಗಿನ ಜಮಾ-ಖರ್ಚು ಮಾಡಿಕೊಂಡು ಶೂನ್ಯ ವರದಿ ಸಲ್ಲಿಸಿರುತ್ತಾರೆ. ಸದರಿ ಸಂಘದ ಅಸ್ತಿತ್ವದಿಂದ ಸದಸ್ಯರಿಗಾಗಲೀ, ಸಾರ್ವಜನಿಕರಿಗಾಗಲೀ ಯಾವುದೇ ಪ್ರಯೋಜನವಿಲ್ಲದಿರುವುದರಿಂದ ಹಾಗೂ ನೋಂದಣಿ ಸಂಖ್ಯೆಯನ್ನು ರದ್ದುಪಡಿಸುವಲ್ಲಿ ಯಾರಿಗೂ ತೊಂದರೆಯಾಗುವುದಿಲ್ಲವೆಂದು ಪರಿಗಣಿಸಿ ಸಮಾಪನಾಧಿಕಾರಿ ಹಾಗೂ ಸಹಕಾರ ಸಂಘಗಳ ಸಹಾಯಕ ನಿಬಂಧಕರು, ಹರಪನಹಳ್ಳಿ ಉಪವಿಭಾಗ, ಹರಪನಹಳ್ಳಿರವರು ಸಂಘದ ನೋಂದಣಿ ರದ್ದತಿಗೆ ಶಿಫಾರಸ್ಸು ಮಾಡಿರುತ್ತಾರೆ. ಈ ಹಿನ್ನೆಲೆಯಲ್ಲಿ ಸಹಕಾರ ಸಂಘಗಳ ಉಪ ನಿಬಂಧಕರು, ದಾವಣಗೆರೆಯವರು ಸದರಿ ಸಂಘದ ನೋಂದಣಿ ರದ್ದತಿಗೆ ಶಿಫಾರಸ್ಸು ಮಾಡಿ ಪ್ರಸ್ತಾವನೆ ಸಲ್ಲಿಸಿರುತ್ತಾರೆ.

ಪ್ರಸ್ತಾವನೆಯನ್ನು ಪರಿಶೀಲಿಸಲಾಗಿದ್ದು, ಸದರಿ ಸಂಘದ ಅಸ್ತಿತ್ವದಿಂದ ಸದಸ್ಯರಿಗಾಗಲೀ, ಸಾರ್ವಜನಿಕರಿಗಾಗಲೀ ಯಾವುದೇ ಪ್ರಯೋಜನವಿಲ್ಲದ್ದರಿಂದ ಹಾಗೂ ಸಂಘದ ನೋಂದಣಿ ಸಂಖ್ಯೆ ರದ್ದುಪಡಿಸುವಲ್ಲಿ ಯಾರಿಗೂ ತೊಂದರೆಯಾಗದೇ ಇರುವುದರಿಂದ, ಸಂಘದ ನೋಂದಣಿ ಸಂಖ್ಯೆಯನ್ನು ರದ್ದುಪಡಿಸುವುದು ಸೂಕ್ತವೆಂದು ಈ ಕೆಳಕಂಡಂತೆ ಆದೇಶಿಸಲಾಗಿದೆ.

**ಆದೇಶ**

**ಸಂ:ಜೆಆರ್‌ಬಿ/ಸಮಾಪನಾ/24/1999-2000, ದಿನಾಂಕ: 30ನೇ ಆಗಸ್ಟ್ 2005**

ಕರ್ನಾಟಕ ಸಹಕಾರ ಸಂಘಗಳ ಕಾಯ್ದೆ 1959ರ ಕಲಂ 75 ರನ್ವಯ ಹಾಗೂ ಸರ್ಕಾರದ ಅಧಿಸೂಚನೆ ಸಂಖ್ಯೆ: ಸಿಎಂಡಬ್ಲ್ಯೂ/09/ಸಿಎಲ್‌ಎಂ/2001, ದಿ:21.11.2001 ರನ್ವಯ ದತ್ತವಾಗಿರುವ ಅಧಿಕಾರವನ್ನು ಚಲಾಯಿಸುತ್ತಾ, ಕೆ.ಹೆಚ್. ತಿಮ್ಮಯ್ಯ, ಸಹಕಾರ ಸಂಘಗಳ ಸಂಯುಕ್ತ ನಿಬಂಧಕರು, ಬೆಂಗಳೂರು ಪ್ರಾಂತ, ಬೆಂಗಳೂರು, ಆದ ನಾನು ಸಮಾಪನೆಯಲ್ಲಿರುವ ಜಗಳೂರು ತಾಲ್ಲೂಕು ಕಲ್ಲುಕುಟ್ಟುವವರ ಮತ್ತು ಮಣ್ಣು ಅಗೆಯುವವರ ಸಹಕಾರ ಸಂಘ ನಿಯಮಿತ, ಜಗಳೂರು ತಾ, ದಾವಣಗೆರೆ ಜಿಲ್ಲೆ, ಇದರ ನೋಂದಣಿ ಸಂಖ್ಯೆ ಡಿಆರ್‌ಡಿ/ಆರ್‌ಎಸ್‌ಆರ್/96/84-85, ದಿನಾಂಕ:25.1.1985 ಅನ್ನು ರದ್ದುಗೊಳಿಸಿ ಈ ಮೂಲಕ ಆದೇಶ ಹೊರಡಿಸಿರುತ್ತೇನೆ. ಈ ರದ್ದತಿಯನ್ವಯ ಸದರಿ ಸಂಘವು ವಿಸರ್ಜಿಸಲ್ಪಟ್ಟಿತೆಂದೂ ಮತ್ತು ಸದರಿ ಸಂಘದ ಅಸ್ತಿತ್ವ ಇಲ್ಲವೆಂದು ಪರಿಗಣಿಸತಕ್ಕದ್ದು. ಈ ಆದೇಶವು ಕೂಡಲೇ ಜಾರಿಗೆ ಬರುವುದು.

ಈ ಆದೇಶವನ್ನು ನನ್ನ ಸ್ವಹಸ್ತಾಕ್ಷರ ಹಾಗೂ ಕಛೇರಿ ಮುದ್ರೆಯೊಂದಿಗೆ ಈ ದಿನ ದಿನಾಂಕ: 30.8.2005 ರಂದು ಹೊರಡಿಸಲಾಗಿದೆ.

**ಕೆ.ಹೆಚ್. ತಿಮ್ಮಯ್ಯ**

ಪಿ.ಆರ್. 1247 ಸಹಕಾರ ಸಂಘಗಳ ಸಂಯುಕ್ತ ನಿಬಂಧಕರು, ಬೆಂಗಳೂರು ಪ್ರಾಂತ, ಬೆಂಗಳೂರು.

**ಸಹಕಾರ ಸಂಘಗಳ ಜಂಟಿ ನಿಬಂಧಕರ ನ್ಯಾಯಾಲಯ, ಬೆಂಗಳೂರು ಪ್ರಾಂತ, ಚಾಮರಾಜಪೇಟೆ, ಬೆಂಗಳೂರು - 560 018**

**ದಾವಾ ಅರ್ಜಿ ಸಂಖ್ಯೆ.ಜೆಆರ್‌ಬಿ:ಡಿಎಸ್:1160:05-06, ದಿನಾಂಕ: 3ನೇ ಸೆಪ್ಟೆಂಬರ್ 2005**

**ವಾದಿ** **ವಿರುದ್ಧ** **ಪ್ರತಿವಾದಿಗಳು**

ಕಲ್ಪವೃಕ್ಷ ಕ್ರೆಡಿಟ್ ಸೌಹಾರ್ದ ಕೋ-ಅಪರೇಟಿವ್ ಲಿಮಿಟೆಡ್
ನಂ.49/1, ಸುಬ್ಬರಾಮಚೆಟ್ಟಿ ರಸ್ತೆ, ನೆಟ್ಟಕಲಪ್ಪ ಸರ್ಕಲ್,
ಬಸವನಗುಡಿ, ಬೆಂಗಳೂರು - 560 004.

1. ಎಂ. ಶೋಭ
ವಯಸ್ಸು 28 ವರ್ಷ ಕೋಂ ಎಸ್. ನಾಗರಾಜ್
ನಂ.1510, 5ನೇ ಅಡ್ಡರಸ್ತೆ, ಕಾರ್ಪೋರೇಷನ್ ಕಾಲೋನಿ,
ಗೋವಿಂದರಾಜನಗರ, ಬೆಂಗಳೂರು - 79
2. ಎಂ. ನಾಗರಾಜ್
ವಯಸ್ಸು 37 ವರ್ಷ ಬಿನ್ ಟಿ. ಮುನಿಯಪ್ಪ
ನಂ.26, ನಾಗರಭಾವಿ ಮುಖ್ಯರಸ್ತೆ, ಗೋವಿಂದರಾಜನಗರ,
ಬೆಂಗಳೂರು-79
3. ಉಮಾ ನಾಗರಾಜ್
ವಯಸ್ಸು 27 ವರ್ಷ ಕೋಂ ಎಂ. ನಾಗರಾಜ್
ನಂ.26, ನಾಗರಭಾವಿ ಮುಖ್ಯರಸ್ತೆ, ಗೋವಿಂದರಾಜನಗರ,
ಬೆಂಗಳೂರು-79.

**1997ರ ಕರ್ನಾಟಕ ಸೌಹಾರ್ದ ಸಹಕಾರಿ ಕಾಯ್ದೆ ಕಲಂ 44ರ ರೀತ್ಯಾ ಸ್ಥಿರಾಸ್ತಿಯನ್ನು ಅಟ್ಯಾಚ್ ಮಾಡಿರುವ ಬಗ್ಗೆ ನೋಟೀಸು**

ವಾದಿಯವರು 1997ರ ಕರ್ನಾಟಕ ಸೌಹಾರ್ದ ಸಹಕಾರಿ ಕಾಯ್ದೆ ಕಲಂ 39 ರನ್ವಯ ಈ ನ್ಯಾಯಾಲಯದ ಮುಂದೆ ಸಲ್ಲಿಸಿರುವ ದಾವಾ ಅರ್ಜಿಯಲ್ಲಿ ಪ್ರತಿವಾದಿಗಳಿಂದ ಒಟ್ಟು ರೂ.6,79,769.00 ಗಳನ್ನು ಶೇಕಡಾ 17 ರಂತೆ ಬಡ್ಡಿ ಮತ್ತು ಶೇ.2 ರಂತೆ ಸುಸ್ತಿ ಬಡ್ಡಿಯೊಂದಿಗೆ ಸಂಪೂರ್ಣ ತೀರುವಳಿಯಾಗುವವರೆಗೆ ವಸೂಲಿ ಮಾಡಲು ಆದೇಶ ನೀಡಬೇಕೆಂದು ಈ ನ್ಯಾಯಾಲಯವನ್ನು ಕೋರಿರುತ್ತಾರೆ. ವಾದಿಯ ಈ ದಾವಾ ಅರ್ಜಿಯನ್ನು ದಾವಾ ನಂ.ಜೆಆರ್‌ಬಿ:ಡಿಎಸ್:1160/05-06 ರನ್ವಯ ಈ ನ್ಯಾಯಾಲಯದ ಕಡತದ ಮೇಲೆ ತೆಗೆದುಕೊಳ್ಳಲಾಗಿದೆ.

ವಾದಿಯು ಅವರ ಈ ದಾವಾ ಅರ್ಜಿಯ ಜೊತೆ 1997ರ ಕರ್ನಾಟಕ ಸೌಹಾರ್ದ ಸಹಕಾರಿ ಕಾಯ್ದೆಯ ಕಲಂ 44 ರನ್ವಯ ಸಲ್ಲಿಸಿರುವ ಅರ್ಜಿಯಲ್ಲಿ ಪ್ರತಿವಾದಿಗಳ ಹೆಸರಿನಲ್ಲಿರುವ ಈ ಕೆಳಗೆ ಷೆಡ್ಯೂಲ್‌ನಲ್ಲಿ ಕಾಣಿಸಿರುವ ಸ್ಥಿರಾಸ್ತಿಯನ್ನು ಮೇಲ್ಕಂಡ ದಾವಾ ಅರ್ಜಿಯಲ್ಲಿ ನೀಡಲಿರುವ ತೀರ್ಪಿಗೆ ಪೂರ್ವ ಜಪ್ತಿ ಮಾಡಿ (Attachment before Judgement) ಆದೇಶ ನೀಡುವಂತೆ ಈ ನ್ಯಾಯಾಲಯವನ್ನು ಕೋರಿರುತ್ತಾರೆ. ಪ್ರತಿವಾದಿಗಳು ಅವರ ಹೆಸರಿನಲ್ಲಿರುವ ಈ ಕೆಳಗೆ ಷೆಡ್ಯೂಲಿನಲ್ಲಿ ಕಾಣಿಸಿರುವ ಸ್ವತ್ತನ್ನು ಮಾರಾಟ ಮಾಡಲು/ಪರಭಾರೆ ಮಾಡಲು ಉದ್ದೇಶಿಸಿದ್ದು ಇದನ್ನು ತಡೆಯದೇ ಇದ್ದಲ್ಲಿ, ವಾದಿಯು ಪ್ರತಿವಾದಿಗಳ ವಿರುದ್ಧ ಹೂಡಿರುವ ದಾವಾ ಅರ್ಜಿಯಲ್ಲಿ ಈ ನ್ಯಾಯಾಲಯವು ಅವಾರ್ಡ್/ಡಿಕ್ರಿ ನೀಡಿದ್ದರೂ ಸದರಿ ಅವಾರ್ಡ್/ಡಿಕ್ರಿಯನ್ವಯ ಪ್ರತಿವಾದಿಗಳಿಂದ ವಾದಿಗೆ ಬರಬೇಕಾದ ಮೊಬಲಗನ್ನು ಪ್ರತಿವಾದಿಗಳಿಂದ ವಸೂಲಿ ಮಾಡಲು ಯಾವುದೇ ರಹವಿಲ್ಲದೇ ಇರುವ ಪರಿಸ್ಥಿತಿ ನಿರ್ಮಾಣವಾಗುವ ಸಾಧ್ಯತೆ ಇದೆ ಎಂದು ಅವರು ಈ ನ್ಯಾಯಾಲಯದ ಗಮನಕ್ಕೆ ತಂದಿರುತ್ತಾರೆ.

ವಾದಿಯ ದಾವಾ ಅರ್ಜಿ ಮತ್ತು ಕಲಂ 44ರ ರೀತ್ಯಾ ಸಲ್ಲಿಸಿರುವ ಅರ್ಜಿಗಳನ್ನು ಕೂಲಂಕುಷವಾಗಿ ಪರಿಶೀಲಿಸಲಾಗಿ, ವಾದಿಯು ಕಲಂ 44 ರ ಅರ್ಜಿಯ ಜೊತೆ ತಿಳಿಸಿರುವ ಅಂಶಗಳು ನಿಜವೆಂಬುದು ಮೇಲ್ನೋಟಕ್ಕೆ ಕಂಡು ಬರುತ್ತದೆ. ಅಲ್ಲದೇ ಪ್ರತಿವಾದಿಗಳು ಈ ಕೆಳಗೆ ಷೆಡ್ಯೂಲ್‌ನಲ್ಲಿ ಕಾಣಿಸಿರುವ ಷೆಡ್ಯೂಲ್ ಸ್ವತ್ತನ್ನು ಮಾರಾಟ ಮಾಡದಂತೆ; ಪರಭಾರೆ ಮಾಡದಂತೆ ತಡೆಯದೇ ಇದ್ದಲ್ಲಿ, ವಾದಿಯ ಈ ದಾವಾ ಅರ್ಜಿಯಲ್ಲಿ ನೀಡಲಿರುವ ಅವಾರ್ಡ್/ಡಿಕ್ರಿಯನ್ನು ಜಾರಿಗೊಳಿಸಲು ಸಾಧ್ಯವಾಗದಂತಹ ಪರಿಸ್ಥಿತಿ ನಿರ್ಮಾಣವಾಗಲಿದೆ. ಎಂಬ ಅಂಶವು ಈ ನ್ಯಾಯಾಲಯಕ್ಕೆ ಸಂಪೂರ್ಣವಾಗಿ ಮನವರಿಕೆಯಾಗಿರುತ್ತದೆ.

ಮೇಲಿನ ಪರಿಸ್ಥಿತಿಯ ಹಿನ್ನೆಲೆಯಲ್ಲಿ ಈ ಕೆಳಕಂಡ ಆದೇಶವನ್ನು ಹೊರಡಿಸಲಾಗಿದೆ.

**ಆದೇಶ**

ಮೇಲೆ ವಿವರಿಸಿರುವ ಪರಿಸ್ಥಿತಿಯ ಹಿನ್ನೆಲೆಯಲ್ಲಿ ಹಾಗೂ 1997ರ ಕರ್ನಾಟಕ ಸೌಹಾರ್ದ ಸಹಕಾರಿ ಕಾಯ್ದೆಯ ಕಲಂ 44 ಹಾಗೂ ಸರ್ಕಾರದ ಅಧಿಸೂಚನೆ ಕ್ರಮಾಂಕ : ಸಿ.ಎಂ.ಡಬ್ಲ್ಯೂ/34/ಸಿಎಲ್‌ಎಂ/2001, ದಿನಾಂಕ:28-2-2003 ರನ್ವಯ ದತ್ತವಾಗಿರುವ ಅಧಿಕಾರವನ್ನು ಚಲಾಯಿಸುತ್ತಾ, ಕೆ.ಹೆಚ್. ತಿಮ್ಮಯ್ಯ, ಸಹಕಾರ ಸಂಘಗಳ ಜಂಟಿ ನಿಬಂಧಕರು, ಬೆಂಗಳೂರು ಪ್ರಾಂತ, ಬೆಂಗಳೂರು ಆದ ನಾನು ಪ್ರತಿವಾದಿಗಳ ಹೆಸರಿನಲ್ಲಿರುವ ಈ ಕೆಳಗೆ ಷೆಡ್ಯೂಲ್‌ನಲ್ಲಿ ಕಾಣಿಸಿರುವ ಸ್ಥಿರಾಸ್ತಿಯನ್ನು ಷರತ್ತಿಗೆ ಒಳಪಟ್ಟು ತೀರ್ಪಿಗೆ ಪೂರ್ವ ಜಪ್ತಿ ಮಾಡಿ ಈ ಮೂಲಕ ಆದೇಶ ನೀಡಿರುತ್ತೇನೆ.

ಪ್ರತಿವಾದಿಗಳು ಒಂದು ವೇಳೆ ಈ ತೀರ್ಪಿಗೆ ಪೂರ್ವಜಪ್ತಿ ಆದೇಶವನ್ನು ಈ ನ್ಯಾಯಾಲಯವು ಹಿಂದಕ್ಕೆ ಪಡೆಯಲು ಇಚ್ಛಿಸಿದಲ್ಲಿ ರೂ.6,79,769.00 ಗಳನ್ನು ವಾದಿಯ ಸಹಕಾರಿ ಸಂಘದಲ್ಲಿ ಅಮಾನತ್ ಖಾತೆಗೆ ಜಮಾ ಮಾಡಿ ದಿನಾಂಕ:6.10.2005 ರ ಒಳಗಾಗಿ ಅಧಿಕೃತ ಚಲನ್ / ರಶೀತಿಯನ್ನು ಈ ನ್ಯಾಯಾಲಯಕ್ಕೆ ಹಾಜರುಪಡಿಸುವಂತೆ ಪ್ರತಿವಾದಿಗಳಿಗೆ ಈ ಮೂಲಕ ನಿರ್ದೇಶಿಸಲಾಗಿದೆ.

ಒಂದು ವೇಳೆ ಪ್ರತಿವಾದಿಗಳು ಮೇಲೆ ತಿಳಿಸಿದಂತೆ ನಿಗದಿತ ದಿನಾಂಕದೊಳಗಾಗಿ ನಗದು ಭದ್ರತೆಯನ್ನು ನೀಡಲು ವಿಫಲರಾದಲ್ಲಿ ಷರತ್ತಿಗೆ ಒಳಪಟ್ಟು ನೀಡಲಾಗಿರುವ ಈ ಅಟ್ಯಾಚ್‌ಮೆಂಟ್ ಆದೇಶವನ್ನು ಸ್ಥಿರೀಕರಿಸಲಾಗುವುದು.

ಈ ಕೆಳಗೆ ಷೆಡ್ಯೂಲ್‌ನಲ್ಲಿ ಕಾಣಿಸಿರುವ ಸ್ಥಿರಾಸ್ಥಿಯನ್ನು ಖರೀದಿಸುವಲ್ಲಿ ಆಸಕ್ತಿ ಹೊಂದಿರುವ ವ್ಯಕ್ತಿಗಳಿಗೆ ಈ ಮೂಲಕ ನೋಟೀಸು ನೀಡಲಾಗಿದ್ದು, ಇವರುಗಳು ಈ ಬಗ್ಗೆ ತೆಗೆದುಕೊಳ್ಳಬಹುದಾದ ಕ್ರಮಕ್ಕೆ ಈ ಅಟ್ಯಾಚ್‌ಮೆಂಟ್ ಆದೇಶವು ಒಳಪಡುತ್ತದೆ ಎಂದು ಈ ಮೂಲಕ ತಿಳಿಯಪಡಿಸಲಾಗಿದೆ.

**ಷೆಡ್ಯೂಲ್ ಆಸ್ತಿಯ ವಿವರ**

ಬೆಂಗಳೂರು ಮಹಾನಗರ ಪಾಲಿಕೆ ವಿಭಾಗ 35ನೇ ವಾರ್ಡ್‌ಗೆ ಸೇರಿದ ಬೆಂಗಳೂರು ನಗರ, ಮಾರೇನಹಳ್ಳಿ 1ನೇ ಮುಖ್ಯರಸ್ತೆಯಲ್ಲಿರುವ ಕಾರ್ಪೋರೇಷನ್ 62ನೇ ನಂಬರುಳ್ಳ ನಿವೇಶನ ಮತ್ತು ಇದರಲ್ಲಿರುವ ಕಟ್ಟಡದ ಸಹಿತವಾದ ಸ್ವತ್ತಿಗೆ ಚಕ್ಕುಬಂದಿ:

ಪೂರ್ವಕ್ಕೆ : 3'0" ಅಡಿ ಪ್ಯಾಸೇಜು ನಂತರ ಬೇರೆಯವರ ಸ್ವತ್ತು
ಪಶ್ಚಿಮಕ್ಕೆ : ಸ್ವತ್ತಿನ ಸಂಖ್ಯೆ 62/2
ಉತ್ತರಕ್ಕೆ : ರಸ್ತೆ
ದಕ್ಷಿಣಕ್ಕೆ : ಬೇರೆಯವರ ಸ್ವತ್ತು

ಈ ಮಧ್ಯೆ ಇರುವ ಪೂರ್ವ-ಪಶ್ಚಿಮ : 25'0" (ಇಪ್ಪತ್ತೈದು ಅಡಿಗಳು), ಉತ್ತರ-ದಕ್ಷಿಣ : 29'0" (ಇಪ್ಪತ್ತೊಂಭತ್ತು ಅಡಿಗಳು), ಒಟ್ಟು : 725'0" ಚದುರ ಅಡಿಗಳು ಮತ್ತು ಪೂರ್ವ-ಪಶ್ಚಿಮ : 37'0" (ಮೂವತ್ತೇಳು ಅಡಿಗಳು), ಉತ್ತರ-ದಕ್ಷಿಣ : ಪೂರ್ವದ ಕಡೆ : 36'0" (ಮೂವತ್ತಾರು ಅಡಿಗಳು), ಪಶ್ಚಿಮದ ಕಡೆ : 45'0" (ನಲವತ್ತೈದು ಅಡಿಗಳು), ಒಟ್ಟು: 1498'5" ಚದುರ ಅಡಿಗಳು ಹಾಗೂ ಪೂರ್ವ-ಪಶ್ಚಿಮ : 22'0" (ಇಪ್ಪತ್ತೆರಡು ಅಡಿಗಳು), ಉತ್ತರ-ದಕ್ಷಿಣ: 25'0" (ಇಪ್ಪತ್ತೈದು ಅಡಿಗಳು), ಒಟ್ಟು 550'0" ಚದುರ ಅಡಿಗಳು, ಒಟ್ಟು ನಿವೇಶನ ವಿಸ್ತೀರ್ಣ : 2773.50 ಚದರ ಅಡಿಗಳು. ಈ ರೀತಿ ಅಳತೆ ಮತ್ತು ಚಕ್ಕುಬಂದಿಗೊಳಪಟ್ಟ ನಿವೇಶನ ಮತ್ತು ಇದರಲ್ಲಿ ಸೈಜುಗಲ್ಲು ಮತ್ತು ಸಿಮೆಂಟ್‌ನಿಂದ ಕಟ್ಟಿರುವ ಪಾಯ, ಸುಟ್ಟ ಇಟ್ಟಿಗೆ ಮತ್ತು ಸಿಮೆಂಟ್‌ನಿಂದ ಕಟ್ಟಿರುವ ಗೋಡೆಗಳು, ಕಾಡುಮರದ ಮತ್ತು ಉಕ್ಕಿನ ಕಿಟಕಿ ಬಾಗಿಲುಗಳು, ಸಿಮೆಂಟ್ ಪ್ಲಾಸ್ಟ್ರಿಂಗ್-ಫ್ಲೋರಿಂಗ್ ಮಾಡಿರುವ ಕಟ್ಟಡ, ಈ ಕಟ್ಟಡಕ್ಕೆ ಸೇರಿದ ಸರ್ವೆ, ಮರ ವಿದ್ಯುತ್ ಸಂಪರ್ಕ, ಕೊಳಾಯಿ ನೀರಿನ ಸಂಪರ್ಕ, ಒಳಚರಂಡಿ ವ್ಯವಸ್ಥೆ ಕಾಂಪೌಂಡು, ವಿದ್ಯುತ್ ಪವರ್ ಸಹಿತವಾದ ಪೂರ್ತಾ ಸ್ಥಿರಸ್ವತ್ತು ಸೇರಿರುತ್ತದೆ.

ಈ ನೋಟೀಸನ್ನು ಈ ದಿನ ದಿನಾಂಕ 3ನೇ ಸೆಪ್ಟೆಂಬರ್ 2005 ರಂದು ನನ್ನ ರುಜು ಹಾಗೂ ಕಛೇರಿಯ ಮೊಹರಿನೊಂದಿಗೆ ನೀಡಲಾಗಿದೆ.

**ಕೆ.ಎಚ್. ತಿಮ್ಮಯ್ಯ**

ಪಿ.ಆರ್. 1248 ಸಹಕಾರ ಸಂಘಗಳ ಜಂಟಿ ನಿಬಂಧಕರು, ಬೆಂಗಳೂರು ಪ್ರಾಂತ, ಬೆಂಗಳೂರು.

## ಸಹಕಾರ ಸಂಘಗಳ ಉಪ ನಿಬಂಧಕರ ಕಛೇರಿ, ಬೀದರ್ ಜಿಲ್ಲೆ, ಬೀದರ್

**ವಿಷಯ:** ಸಮಾಪನೆಗೊಂಡಿರುವ ಹಾಲು ಉತ್ಪಾದಕರ ಸಹಕಾರ ಸಂಘ ನಿ. ಎಕಲೂರು ತಾ: ಬಸವಕಲ್ಯಾಣ ಇದರ ನೋಂದಣಿ ಸಂಖ್ಯೆ ರದ್ದುಪಡಿಸುವ ಕುರಿತು.

**ಉಲ್ಲೇಖ:**
1. ಈ ಕಛೇರಿ ಆದೇಶ ಸಂಖ್ಯೆ:ಉನಿಬಿ/ವಿ1/ಸಮಾಪನೆ/98-1999 ದಿನಾಂಕ: 17.11.1998.
2. ಸಹಕಾರ ಸಂಘಗಳ ಸಹಾಯಕ ನಿಬಂಧಕರು, ಬೀದರ್ ಉಪ ವಿಭಾಗ, ಬೀದರ್ ಇವರ ಪತ್ರ ಸಂಖ್ಯೆ/ಸನಿಬಿ1/ವಿ6/ಸಮಾಪನೆ/ಸಿಆರ್- /2003-2004/ದಿನಾಂಕ 22.12.2003 ಹಾಗೂ 16.8.2005.

**ಪ್ರಸ್ತಾವನೆ:**

ಹಾಲು ಉತ್ಪಾದಕರ ಸಹಕಾರ ಸಂಘ ನಿ, ಎಕಲೂರು ತಾ: ಬಸವಕಲ್ಯಾಣ ಈ ಸಂಘವು ಸಂಖ್ಯೆ/ಎಆರ್-1 ಎಸ್-3/ಜೆಓಟಿ/18282/1992-93 ದಿನಾಂಕ:28.1.93 ರಲ್ಲಿ ನೊಂದಣಿಯಾಗಿರುತ್ತದೆ. ಸಂಘದ ಕಾರ್ಯ ಚಟುವಟಿಕೆಗಳು ಪೂರ್ಣ ಸ್ಥಗಿತಗೊಂಡಿದ್ದರಿಂದ ಈ ಸಂಘವನ್ನು ಮುಂದುವರಿಸಿಕೊಂಡು ಹೋಗುವುದು ಸೂಕ್ತವಲ್ಲವೆಂದು ಭಾವಿಸಿ, ಉಲ್ಲೇಖ (1)ರ ಆದೇಶದಲ್ಲಿ ಸಮಾಪನೆಗೊಳಿಸಿ ಮಾರ್ಗ ವಿಸ್ತೀರ್ಣಾಧಿಕಾರಿ ಕೆ.ಎಂ.ಎಫ್. ಇವರನ್ನು ಸಮಾಪನಾಧಿಕಾರಿಯನ್ನಾಗಿ ನೇಮಕ ಮಾಡಲಾಗಿತ್ತು. ಸಮಾಪನಾಧಿಕಾರಿಗಳು ಸಂಘದ ನೊಂದಣಿ ಸಂಖ್ಯೆ ರದ್ದುಪಡಿಸಲು ಸಹಕಾರ ಸಂಘಗಳ ಸಹಾಯಕ ನಿಬಂಧಕರು, ಬೀದರ್ ಇವರ ಮೂಲಕ ಉಲ್ಲೇಖ (2)ರ ಮುಖೇನ ಪ್ರಸ್ತಾವನೆ ಸಲ್ಲಿಸಿರುತ್ತಾರೆ. ಸಹಕಾರ ಸಂಘಗಳ ಸಹಾಯಕ ನಿಬಂಧಕರು, ಬೀದರ್ ಇವರು ಸಂಘದಲ್ಲಿ ಯಾವುದೇ ಆಸ್ತಿ-ಜವಾಬ್ದಾರಿ ಇರುವುದಿಲ್ಲ ಮತ್ತು ಸಂಘದಿಂದ ಸರ್ಕಾರಕ್ಕೆ ಬರಬೇಕಾದ ಯಾವುದೇ ಬಾಕಿ ಇಲ್ಲವೆಂದು ಪ್ರಮಾಣ ಪತ್ರ ನೀಡಿರುತ್ತಾರೆ. ಹಾಗೂ ಸಂಘದ ಹೆಸರಿನಲ್ಲಿ ಇರುವ ಶಿಲ್ಕು ಹಣವನ್ನು ಉಪ ನಿಬಂಧಕರ ಪಿ.ಡಿ. ಖಾತೆಗೆ ವರ್ಗಾಯಿಸಿ ಸಂಘದ ನೊಂದಣಿ ಸಂಖ್ಯೆ ರದ್ದುಪಡಿಸಲು ಶಿಫಾರಸ್ಸು ಮಾಡಿರುತ್ತಾರೆ. ಈ ಅಂಶಗಳನ್ನು ಪರಿಗಣಿಸಿ ಕೆಳಕಂಡ ಆದೇಶ ಹೊರಡಿಸಲಾಗಿದೆ.

### ಆದೇಶ

### ಸಂಖ್ಯೆ/ಉನಿಬಿ/ವಿ2/ಸಮಾಪನೆ/ಸಿಆರ್- /2005-2006/2221, ದಿನಾಂಕ: 30ನೇ ಆಗಸ್ಟ್ 2005

ಪ್ರಸ್ತಾವನೆಯಲ್ಲಿನ ಅಂಶಗಳನ್ನು ಪರಿಗಣಿಸಿ, ಕರ್ನಾಟಕ ಸಹಕಾರ ಸಂಘಗಳ ಕಾಯ್ದೆ 1959ರ ಕಲಂ 75 ರನ್ವಯ ಹಾಗೂ ಸರ್ಕಾರಿ ಅಧಿಸೂಚನೆ ಸಂಖ್ಯೆ ಸಿಎಂಡಬ್ಲ್ಯೂ/69/ಸಿಎಲ್‌ಎಂ/200/ದಿನಾಂಕ:21.11.2001 ರಲ್ಲಿ ದತ್ತವಾಗಿರುವ ಅಧಿಕಾರವನ್ನು ಚಲಾಯಿಸುತ್ತಾ **ಎಂ.ಡಿ. ಮಠಪತಿ** ಸಹಕಾರ ಸಂಘಗಳ ಉಪ ನಿಬಂಧಕರು, ಬೀದರ್ ಜಿಲ್ಲೆ ಬೀದರ್ ಆದ ನಾನು ಸಮಾಪನೆಗೊಂಡ ಹಾಲು ಉತ್ಪಾದಕರ ಸಹಕಾರ ಸಂಘ ನಿ, **ಎಕಲೂರು ತಾ: ಬಸವಕಲ್ಯಾಣ** ಇದರ ನೊಂದಣಿ **ಸಂಖ್ಯೆ/ಎಆರ್-1/ಎಸ್.3/ಜೆಓಟಿ/18282/1992-93** ದಿನಾಂಕ:28.1.93 ನ್ನು ರದ್ದುಗೊಳಿಸಿ ಆದೇಶ ಹೊರಡಿಸಿರುತ್ತೇನೆ.

ಈ ರದ್ದತಿಯ ಆದೇಶದ ದಿನಾಂಕದಿಂದ ಸದರಿ ಸಹಕಾರ ಸಂಘದ ಕಾರ್ಯಾಚಟುವಟಿಕೆಗಳು ನಿಂತುಹೋಗಿರುತ್ತವೆಂದು ಭಾವಿಸತಕ್ಕದ್ದು. ಈ ಸಂಘವು ಅಸ್ತಿತ್ವದಲ್ಲಿರುವುದಿಲ್ಲವೆಂದು ಪರಿಗಣಿಸತಕ್ಕದ್ದು. ಹಾಗೂ ಕರ್ನಾಟಕ ಸಹಕಾರ ಸಂಘಗಳ ನಿಯಮಗಳ 1960ರ ನಿಯಮ 33 (ಎನ್) ರನ್ವಯ ಈ ಸಂಘದ ದಾಖಲಾತಿಗಳನ್ನು ಸಹಕಾರ ಸಂಘಗಳ ಸಹಾಯಕ ನಿಬಂಧಕರು, ಬೀದರ್ ಇವರ ಕಛೇರಿಯಲ್ಲಿಡಲು ಆದೇಶಿಸಿದೆ.

ನನ್ನ ಸ್ವ ಸಹಿ ಮತ್ತು ಈ ಕಛೇರಿ ಮುದ್ರೆಯೊಂದಿಗೆ ದಿನಾಂಕ: 30.8.2005 ರಂದು ಈ ಆದೇಶವನ್ನು ಹೊರಡಿಸಲಾಗಿದೆ.

ಪಿ.ಆರ್. 1249 ಸಹಕಾರ ಸಂಘಗಳ ಉಪ ನಿಬಂಧಕರು, ಬೀದರ್.

## ಸಹಕಾರ ಸಂಘಗಳ ಉಪ ನಿಬಂಧಕರ ಕಛೇರಿ, ಬೀದರ್ ಜಿಲ್ಲೆ, ಬೀದರ್

**ವಿಷಯ:** ಸಮಾಪನೆಗೊಂಡ ಮಾಂಜರಾ ಹಾಲು ಉತ್ಪಾದಕರ ಸಹಕಾರ ಸಂಘ ನಿ, ಠಾಣಾಕುಶನೂರ ತಾ: ಔರಾದ ಇದರ ನೊಂದಣಿ ಸಂಖ್ಯೆ ರದ್ದುಪಡಿಸುವ ಕುರಿತು.

**ಉಲ್ಲೇಖ:**
1. ಈ ಕಛೇರಿ ಆದೇಶ ಸಂಖ್ಯೆ/ಡಿಆರ್‌ಎಫ್/ಎಲ್‌ಬಿಎಸ್/87-88 ದಿನಾಂಕ: 12.11.1987.
2. ಕಾಮಧೇನು ಯೋಜನೆ ವಿಮರ್ಶೆ ಸಭೆ ನಡವಳಿಕೆ ಪತ್ರ ಸಂಖ್ಯೆ/ಜಿಪಿಬಿ/ಡಿಆರ್‌ಡಿಎ/ಕಾಮಧೇನು/ಸಿಆರ್-60/2003-2004 ದಿನಾಂಕ 22.7.2005.
3. ಸಹಕಾರ ಅಭಿವೃದ್ಧಿ ಅಧಿಕಾರಿ, ಭಾಲ್ಕಿ ಇವರ ಪತ್ರ ದಿನಾಂಕ 29.1.05
4. ಸಹಕಾರ ಸಂಘಗಳ ಸಹಾಯಕ ನಿಬಂಧಕರು, ಬೀದರ್ ಇವರ ಪ್ರಸ್ತಾವನೆ ಸಂಖ್ಯೆ/ಸನಿಬಿ1/ವಿ2/ಸಮಾಪನೆ/ಸಿಆರ್-35/2005-2006/ದಿನಾಂಕ 9.6.2005.

**ಪ್ರಸ್ತಾವನೆ:**

ಮಾಂಜರಾ ಹಾಲು ಉತ್ಪಾದಕರ ಸಹಕಾರ ಸಂಘ ನಿ, ಠಾಣಾಕುಶನೂರ ತಾ: ಔರಾದ ಈ ಸಂಘವು ಸಂಖ್ಯೆ/99/ಎಆರ್‌ಆರ್/ಬಿಡಿಆರ್/1966-67/ದಿನಾಂಕ:25.5.1967 ರಲ್ಲಿ ನೊಂದಣಿ ಆಗಿರುತ್ತದೆ. ಸಂಘದ ಕಾರ್ಯಚಟುವಟಿಕೆಗಳು ಸಂಪೂರ್ಣವಾಗಿ ಸ್ಥಗಿತಗೊಂಡಿದ್ದರಿಂದ ಇದನ್ನು ಸಮಾಪನೆಗೊಳಿಸಿ ಕ್ಷೇತ್ರ ಸಹಾಯಕರು, ಡಿಸಿಸಿ ಬ್ಯಾಂಕ್ ಶಾಖೆ, ಠಾಣಾಕುಶನೂರ ಇವರಿಗೆ ಸಮಾಪನಾಧಿಕಾರಿಯನ್ನಾಗಿ ನೇಮಿಸಿ ಸಂಘದ ಆಸ್ತಿ ಜವಾಬ್ದಾರಿ ವಿಲೇಗೊಳಿಸಲು ಹಾಗೂ ನೊಂದಣಿ ರದ್ದತಿಗೆ ಪ್ರಸ್ತಾವನೆ ಸಲ್ಲಿಸಲು ಉಲ್ಲೇಖ (1) ರಲ್ಲಿ ಸೂಚಿಸಲಾಗಿತ್ತು.

ಮುಂದುವರೆದು, ಸಂಘದ ಯಾವುದೇ ದಾಖಲಾತಿ ಪುಸ್ತಕಗಳು ಲಭ್ಯವಿರುವುದಿಲ್ಲವೆಂಬುದನ್ನು ಪರಿಶೀಲಿಸಲಾಗಿ ಸಂಘಕ್ಕೆ ಬಹಳ ವರ್ಷಗಳ ಹಿಂದೆ ಊರು ಗೈರಾಣ ಜಮೀನು ಹಂಚಿಕೆ ಮಾಡಲಾಗಿದೆ ಎಂದು ತಿಳಿದು ಬಂದ ಪ್ರಯುಕ್ತ ದಿನಾಂಕ:10.10.98 ರಂದು ಸದರಿ ಗ್ರಾಮದ ಪ್ರಮುಖರು ಪಂಚನಾಮಾ ಮಾಡಿ ನಿವೇಶನ (48' x 42' ಅಳತೆಯ) ದಲ್ಲಿ ಸುಮಾರು 10' x 10' ಅಳತೆಯ ಒಂದು ಹಳೆ ಕಟ್ಟಡ ಇರುತ್ತದೆ ಎಂದು ತಿಳಿಸಿರುವುದನ್ನು ಉಲ್ಲೇಖ (3) ರಲ್ಲಿ ವರದಿಯಾಗಿರುತ್ತದೆ.

ಉಲ್ಲೇಖ (2)ರ ಕಾಮಧೇನು ಯೋಜನೆ ವಿಮರ್ಶೆ ಸಭೆ ನಡವಳಿಕೆಗಳ ಪ್ರಕಾರ ಸದರಿ ನಿವೇಶನ (ಜಮೀನು) ವನ್ನು ಕೆ.ಎಂ.ಎಫ್. ಗೆ ವಹಿಸಿಕೊಡಲು ತಿಳಿಸಲಾದ ಹಿನ್ನೆಲೆಯಲ್ಲಿ, ಸಂಘದಿಂದ ಸರ್ಕಾರಕ್ಕೆ ಹಾಗೂ ಡಿಸಿಸಿ ಬ್ಯಾಂಕಿಗೆ ಬರಬೇಕಾದ ಸಾಲವನ್ನು ಕೆ.ಎಂ.ಎಫ್. ನಿಂದ ಭರಿಸಲಾಗಿದೆ. ಹಾಗೂ ಇತರೆ ಯಾವುದೇ ಜವಾಬ್ದಾರಿಗಳಿದ್ದಲ್ಲಿ ಕೆ.ಎಂ.ಎಫ್. ಗುಲ್ಬರ್ಗಾ/ಬೀದರ್ ಕ್ಕೆ ವರ್ಗಾಯಿಸಿ ನೊಂದಣಿ ಸಂಖ್ಯೆ ರದ್ದುಪಡಿಸಲು ಸಮಾಪನಾಧಿಕಾರಿಗಳು ತಮ್ಮ ಅಂತಿಮ ಸಮಾಪನೆ ನಡವಳಿಕೆಗಳಲ್ಲಿ ತೀರ್ಮಾನಿಸಿ ಪ್ರಸ್ತಾವನೆ ಸಲ್ಲಿಸಿರುವುದನ್ನು ಸಹಕಾರ ಸಂಘಗಳ ಸಹಾಯಕ ನಿಬಂಧಕರು, ಬೀದರ್‌ರವರು ಸಹ ಶಿಫಾರಸ್ಸು ಮಾಡಿರುತ್ತಾರೆ.

ಈ ಅಂಶಗಳನ್ನು ಪರಿಗಣಿಸಿ ಸದರಿ ಸಂಘದ ನಿವೇಶನ ಹಾಗೂ ಕಟ್ಟಡದಲ್ಲಿ ಕೆ.ಎಂ.ಎಫ್. ಬೀದರ ಶಾಖೆಯ ವತಿಯಿಂದ ಶಿಥಲ ಗೃಹ ನಿರ್ಮಾಣ ಮಾಡಲು ಆ ನಿವೇಶನ/ಕಟ್ಟಡದೊಂದಿಗೆ ಸಂಘದ ಎಲ್ಲಾ ಆಸ್ತಿ - ಜವಾಬ್ದಾರಿಗಳು ಕೆ.ಎಂ.ಎಫ್.ಗೆ ವರ್ಗಾಯಿಸಿ ಕೆಳಕಂಡ ಆದೇಶ ಹೊರಡಿಸಲಾಗಿದೆ.

**ಆದೇಶ**

**ಸಂಖ್ಯೆ/ಉನಿಬಿ/ವಿ2/ಸಮಾಪನೆ/ಸಿಆರ್- /2005-2006/2235, ದಿನಾಂಕ: 30ನೇ ಆಗಸ್ಟ್ 2005**

ಪ್ರಸ್ತಾವನೆಯಲ್ಲಿನ ಅಂಶಗಳನ್ನು ಪರಿಗಣಿಸಿ, ಕರ್ನಾಟಕ ಸಹಕಾರ ಸಂಘಗಳ ಕಾಯ್ದೆ 1959ರ ಕಲಂ 75 ರನ್ವಯ ಹಾಗೂ ಸರ್ಕಾರಿ ಅಧಿಸೂಚನೆ ಸಂಖ್ಯೆ ಸಿಎಂಡಬ್ಲ್ಯೂ/69/ಸಿಎಲ್‌ಎಂ/200/ದಿನಾಂಕ:21.11.2001 ರಲ್ಲಿ ದತ್ತವಾಗಿರುವ ಅಧಿಕಾರವನ್ನು ಚಲಾಯಿಸುತ್ತಾ **ಎಂ.ಡಿ. ಮಠಪತಿ** ಸಹಕಾರ ಸಂಘಗಳ ಉಪ ನಿಬಂಧಕರು, ಬೀದರ್ ಜಿಲ್ಲೆ ಬೀದರ್ ಆದ ನಾನು ಸಮಾಪನೆಗೊಂಡ ಮಾಂಜಾರಾ ಹಾಲು ಉತ್ಪಾದಕರ ಸಹಕಾರ ಸಂಘ ನಿ, **ಠಾಣಾಕುಶನೂರ ತಾ: ಔರಾದ** ಇದರ ನೊಂದಣಿ ಸಂಖ್ಯೆ/99/ಎಆರ್‌ಆರ್/ಬಿಡಿಆರ್/1966-67/ದಿನಾಂಕ:25.5.1967 ನ್ನು ರದ್ದುಗೊಳಿಸಿ ಆದೇಶ ಹೊರಡಿಸಿರುತ್ತೇನೆ.

ಈ ರದ್ದತಿಯ ಆದೇಶದ ದಿನಾಂಕದಿಂದ ಸದರಿ ಸಹಕಾರ ಸಂಘದ ಕಾರ್ಯಚಟುವಟಿಕೆಗಳು ನಿಂತುಹೋಗಿರುತ್ತವೆಂದು ಭಾವಿಸತಕ್ಕದ್ದು. ಹಾಗೂ ಈ ಸಂಘವು ಅಸ್ತಿತ್ವದಲ್ಲಿರುವುದಿಲ್ಲವೆಂದು ಪರಿಗಣಿಸತಕ್ಕದ್ದು. ಹಾಗೂ ಸದರಿ ಸಂಘದ ಯಾವುದೇ ಆಸ್ತಿ-ಜವಾಬ್ದಾರಿ ಇದ್ದಲ್ಲಿ ಅದನ್ನು ಗುಲ್ಬರ್ಗಾ ಬೀದರ್ ಹಾಲು ಉತ್ಪಾದಕರ ಸಹಕಾರ ಸಂಘಗಳ ಮಹಾ ಮಂಡಳ ನಿಯಮಿತ ಗುಲ್ಬರ್ಗಾಕ್ಕೆ ವರ್ಗಾಯಿಸಲಾಗಿದೆ. ಮಹಾ ಮಂಡಳದ ಲೆಕ್ಕ ಪರಿಶೋಧನಾ ವೇಳೆಯಲ್ಲಿ ಸದರಿ ಸಂಘದ ಆಸ್ತಿ - ಜವಾಬ್ದಾರಿಗಳನ್ನು ಪ್ರತ್ಯೇಕವಾಗಿ ಮಹಾ ಮಂಡಳದ ಆಸ್ತಿ - ಜವಾಬ್ದಾರಿ ತಃಖ್ತೆಯಲ್ಲಿ ಸೇರಿಸಿಕೊಳ್ಳುವುದು.

ನನ್ನ ಸ್ವ ಸಹಿ ಮತ್ತು ಈ ಕಛೇರಿ ಮುದ್ರೆಯೊಂದಿಗೆ ದಿನಾಂಕ: 30.8.2005 ರಂದು ಈ ಆದೇಶವನ್ನು ಹೊರಡಿಸಲಾಗಿದೆ.

ಪಿ.ಆರ್. 1250 ಸಹಕಾರ ಸಂಘಗಳ ಉಪ ನಿಬಂಧಕರು, ಬೀದರ್.

**ಸಹಕಾರ ಸಂಘಗಳ ಸಂಯುಕ್ತ ನಿಬಂಧಕರು, ಬೆಂಗಳೂರು ಪ್ರಾಂತ, ಬೆಂಗಳೂರು**

**ವಿಷಯ:** ತುಂಗಾ ಗೃಹ ನಿರ್ಮಾಣ ಸಹಕಾರ ಸಂಘ ನಿಯಮಿತ, ತೀರ್ಥಹಳ್ಳಿ, ಇದರ ಸಮಾಪನೆಗೊಳಿಸುವ ಬಗ್ಗೆ.

**ಉಲ್ಲೇಖ:** ಸಹಕಾರ ಸಂಘಗಳ ಉಪ ನಿಬಂಧಕರು, ಶಿವಮೊಗ್ಗ ರವರ ಪ್ರಸ್ತಾವೆ ಸಂ:ಡಿಆರ್‌ಎಸ್:ಸಮಾಪನೆ:477:2005-06, ದಿನಾಂಕ: 28.6.2005

**ಪ್ರಸ್ತಾವನೆ:**

ತುಂಗಾ ಗೃಹ ನಿರ್ಮಾಣ ಸಹಕಾರ ಸಂಘ ನಿಯಮಿತ, ತೀರ್ಥಹಳ್ಳಿ, ಶಿವಮೊಗ್ಗ ಈ ಸಹಕಾರ ಸಂಘವು ನೋಂದಣಿ ಸಂ:ಜೆಡಿಆರ್‌ಎಸ್: ಆರ್‌ಇಬಿಎಸ್:97:72-73, ದಿನಾಂಕ:5.3.1972 ರಲ್ಲಿ ನೋಂದಣಿಯಾಗಿದ್ದು, ಸಂಘದ ಕಾರ್ಯವ್ಯಾಪ್ತಿಯು ತಾಲ್ಲೂಕು ಮಟ್ಟದ್ದಾಗಿರುತ್ತದೆ. ಸಂಘದ ಆಡಳಿತ ಮಂಡಳಿಯು ನಿಗದಿತ ಅವಧಿಯಲ್ಲಿ 2005-06 ರಿಂದ 2009-10 ರವರೆಗಿನ 5 ಸಹಕಾರ ವರ್ಷಗಳಿಗೆ ಚುನಾವಣೆಯನ್ನು ನಡೆಸಲು ವಿಫಲವಾದ ಪ್ರಯುಕ್ತ ಸಹಕಾರ ಸಂಘಗಳ ಉಪ ನಿಬಂಧಕರು, ಶಿವಮೊಗ್ಗ ರವರ ಆದೇಶದ ದಿನಾಂಕ: 1.4.2005 ರನ್ವಯ ಸಹಕಾರ ಅಭಿವೃದ್ಧಿ ಅಧಿಕಾರಿ, ತೀರ್ಥಹಳ್ಳಿ, ಇವರನ್ನು ಆಡಳಿತಾಧಿಕಾರಿಯಾಗಿ ನೇಮಿಸಿದ್ದು, ಸದರಿಯವರು ದಿನಾಂಕ: 24.4.2005 ರಂದು ಪ್ರಭಾರ ವಹಿಸಿಕೊಂಡು, ದಿನಾಂಕ: 12.5.2005 ರಂದು ಆಡಳಿತಾಧಿಕಾರಿ ಸಭೆ ನಡೆಸಿದ್ದು, ಸಂಘವು 3 ವರ್ಷಗಳಿಂದ ವ್ಯವಹಾರವನ್ನು ನಡೆಸದ ಪ್ರಯುಕ್ತ ಸಂಘಕ್ಕೆ ಯಾವುದೇ ಆದಾಯ ಇಲ್ಲದ್ದರಿಂದ ಸಂಘವು ಬೈಲಾ ರೀತ್ಯಾ ಕಾರ್ಯಚಟುವಟಿಕೆಗಳನ್ನು ನಡೆಸಲು ಸಾಧ್ಯವಾಗುತ್ತಿಲ್ಲ. ಸಂಘದ 9 ಜನ ಸದಸ್ಯರಿಂದಾದ ಸುಸ್ತಿ ಸಾಲ ಒಟ್ಟು ರೂ.5,83,729-00 ಗಳು ವಸೂಲಾಗಬೇಕಿರುತ್ತದೆ. ಸಂಘದ 2001-02ನೇ ಸಾಲಿನ ಲೆಕ್ಕ ಪತ್ರಗಳು ಲೆಕ್ಕ ತಪಾಸಣೆ ಆಗಿರುವುದಿಲ್ಲ. ಹಾಗೂ ಸಂಘದ ವ್ಯವಹಾರವನ್ನು ಮುಂದುವರೆಸಿಕೊಂಡು ಹೋಗಲು ಯಾವ ಸದಸ್ಯರಿಗೂ ಆಸಕ್ತಿ ಇರುವುದಿಲ್ಲ. ಈ ಎಲ್ಲಾ ಅಂಶಗಳ ಹಿನ್ನೆಲೆಯಲ್ಲಿ ಸಹಕಾರ ಸಂಘಗಳ ಸಹಾಯಕ ನಿಬಂಧಕರು, ಶಿವಮೊಗ್ಗ ಹಾಗೂ ಸಹಕಾರ ಸಂಘಗಳ ಉಪ ನಿಬಂಧಕರು, ಶಿವಮೊಗ್ಗರವರು ಈ ಸಂಘವನ್ನು ಸಮಾಪನೆಗೊಳಿಸಲು ಶಿಫಾರಸ್ಸು ಮಾಡಿ ಪ್ರಸ್ತಾವೆ ಸಲ್ಲಿಸಿರುತ್ತಾರೆ.

ಪ್ರಸ್ತಾವೆಯನ್ನು ಪರಿಶೀಲಿಸಲಾಗಿದ್ದು, ಸಂಘದವರಿಗೆ ಸಂಘದ ವ್ಯವಹಾರವನ್ನು ಮುಂದುವರೆಸಿಕೊಂಡು ಹೋಗಲು ಆಸಕ್ತಿ ಇಲ್ಲದಿರುವುದನ್ನು ಗಮನಿಸಲಾಗಿದ್ದು, ಸಂಘದ ಪುನಃಶ್ಚೇತನ ಸಾಧ್ಯವಿಲ್ಲದಿರುವುದರಿಂದ ಸಂಘವನ್ನು ಸಮಾಪನೆಗೊಳಿಸುವುದೇ ಸೂಕ್ತವೆಂದು ಈ ಕೆಳಕಂಡಂತೆ ಆದೇಶಿಸಲಾಗಿದೆ.

## ಆದೇಶ

**ಸಂಖ್ಯೆ: ಜೆಆರ್‌ಬಿ:ಎಲ್‌ಕ್ಯೂಡಿ:06:ಎಲ್‌ಎಂಸಿ:2005-06, ದಿನಾಂಕ: 29ನೇ ಆಗಸ್ಟ್ 2005**

ಕರ್ನಾಟಕ ಸಹಕಾರ ಸಂಘಗಳ ಕಾಯ್ದೆ 1959ರ ಕಲಂ 72(2) ರನ್ವಯ ಹಾಗೂ ಸರ್ಕಾರದ ಅಧಿಸೂಚನೆ ಸಂಖ್ಯೆ: ಸಿಎಂಡಬ್ಲ್ಯೂ:09: ಸಿಎಲ್‌ಎಂ:2001, ದಿನಾಂಕ:21.11.2001 ರನ್ವಯ ದತ್ತವಾಗಿರುವ ಅಧಿಕಾರವನ್ನು ಚಲಾಯಿಸುತ್ತಾ, ಕೆ.ಹೆಚ್. ತಿಮ್ಮಯ್ಯ, ಸಹಕಾರ ಸಂಘಗಳ ಸಂಯುಕ್ತ ನಿಬಂಧಕರು, ಬೆಂಗಳೂರು ಪ್ರಾಂತ, ಬೆಂಗಳೂರು ಆದ ನಾನು ತುಂಗಾ ಗೃಹ ನಿರ್ಮಾಣ ಸಹಕಾರ ಸಂಘ ನಿಯಮಿತ, ತೀರ್ಥಹಳ್ಳಿ, ಶಿವಮೊಗ್ಗ ಜಿಲ್ಲೆ ಈ ಸಹಕಾರ ಸಂಘವನ್ನು ಈ ಕೂಡಲೇ ಜಾರಿಗೆ ಬರುವಂತೆ ಸಮಾಪನೆಗೊಳಿಸಿ, ಕಲಂ 73 ರನ್ವಯ ಸಹಕಾರ ಅಭಿವೃದ್ಧಿ ಅಧಿಕಾರಿ, ತೀರ್ಥಹಳ್ಳಿ ಇವರನ್ನು ಸಮಾಪನಾಧಿಕಾರಿಯನ್ನಾಗಿ ನೇಮಿಸಿ ಆದೇಶಿಸಿರುತ್ತೇನೆ.

ನೇಮಕಗೊಂಡ ಸಮಾಪನಾಧಿಕಾರಿಯು ಸಂಘದ ಪ್ರಭಾರವನ್ನು ಕೂಡಲೇ ಪಡೆದುಕೊಂಡು ಸಂಘದ ಆಸ್ತಿ-ಜವಾಬ್ದಾರಿಯನ್ನು ರದ್ದುಪಡಿಸಲು ಈ ಆದೇಶದ ದಿನಾಂಕದಿಂದ 90 (ತೊಂಭತ್ತು) ದಿನಗಳೊಳಗಾಗಿ ಪ್ರಸ್ತಾವೆಯನ್ನು ಸಲ್ಲಿಸತಕ್ಕದ್ದು.

ಈ ಆದೇಶವನ್ನು ನನ್ನ ಸ್ವಹಸ್ತಾಕ್ಷರ ಹಾಗೂ ಕಛೇರಿ ಮುದ್ರೆಯೊಂದಿಗೆ ಈ ದಿನ ದಿನಾಂಕ 29.8.2005 ರಂದು ಹೊರಡಿಸಲಾಗಿದೆ.

ಪಿ.ಆರ್. 1251 ಸಹಕಾರ ಸಂಘಗಳ ಸಂಯುಕ್ತ ನಿಬಂಧಕರು, ಬೆಂಗಳೂರು ಪ್ರಾಂತ, ಬೆಂಗಳೂರು.

## ವಾಣಿಜ್ಯ ಮತ್ತು ಕೈಗಾರಿಕೆ ಇಲಾಖೆ

**ಅಧಿಸೂಚನೆ ಸಂಖ್ಯೆ: ವಾಕೈ 16 ಜಕೈಸೇ 2004, ಬೆಂಗಳೂರು, ದಿನಾಂಕ: 24ನೇ ಆಗಸ್ಟ್ 2005**

**ವಿಷಯ:** ಕೈಮಗ್ಗ ಮತ್ತು ಜವಳಿ ಇಲಾಖೆಯ ಜವಳಿ ಪ್ರವರ್ಧನಾಧಿಕಾರಿಗಳ ಅಂತಿಮ ಜೇಷ್ಠತಾ ಪಟ್ಟಿ ಬಗ್ಗೆ.

ಕೈಮಗ್ಗ ಮತ್ತು ಜವಳಿ ಇಲಾಖೆಯ ಜವಳಿ ಪ್ರವರ್ಧನಾಧಿಕಾರಿಗಳ ವೃಂದದ ಕರಡು ಜೇಷ್ಠತಾ ಪಟ್ಟಿಯನ್ನು ದಿನಾಂಕ:1.6.2005ರಂದು ಇದ್ದಂತೆ ಸರ್ಕಾರಿ ಅಧಿಸೂಚನೆ ಸಂಖ್ಯೆ:ವಾಕೈ 16 ಜಕೈಸೇ 2004, ದಿನಾಂಕ: 6.6.2005ರಲ್ಲಿ ಪ್ರಕಟಿಸಲಾಗಿತ್ತು. ಆ ಕುರಿತಂತೆ ಕರಡು ಜೇಷ್ಠತಾ ಪಟ್ಟಿಯ ಬಗ್ಗೆ ಪಡೆಯಲಾಗಿದ್ದ ಆಕ್ಷೇಪಣೆಗಳನ್ನು ನಿಯಮಾನುಸಾರ ಪರಿಶೀಲಿಸಲಾಗಿದೆ. ಅದರಂತೆ ಆಕ್ಷೇಪಣೆಗಳಲ್ಲಿ ಯಾವುದೇ ಸಮರ್ಥನಾ ಕಾರಣಗಳು ಕಂಡು ಬಾರದ ಕಾರಣ ದಿನಾಂಕ: 6.6.2005ರಂದು ಹೊರಡಿಸಿದ ಕರಡು ಅಧಿಸೂಚನೆಯನ್ನು ಅಂತಿಮ ಜೇಷ್ಠತಾ ಪಟ್ಟಿಯನ್ನಾಗಿ ಪರಿಗಣಿಸಿ ಈ ಅಧಿಸೂಚನೆಯ ಅನುಬಂಧ-1ರಲ್ಲಿ ನಮೂದಿಸಿರುವಂತೆ ಅಂತಿಮ ಜೇಷ್ಠತಾ ಪಟ್ಟಿಯನ್ನು ಪ್ರಕಟಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

**ಕೆ.ಎಲ್. ಜಯರಾಮ್**

ಸರ್ಕಾರದ ಉಪ ಕಾರ್ಯದರ್ಶಿ, ವಾಣಿಜ್ಯ ಮತ್ತು ಕೈಗಾರಿಕೆ ಇಲಾಖೆ.

### ಅನುಬಂಧ-1

**ದಿನಾಂಕ:1.6.2005ಕ್ಕೆ ಇದ್ದಂತೆ ಕೈಮಗ್ಗ ಮತ್ತು ಜವಳಿ ಇಲಾಖೆಯ ಜವಳಿ ಪ್ರವರ್ಧನಾಧಿಕಾರಿಗಳ ಅಂತಿಮ ಜೇಷ್ಠತಾ ಪಟ್ಟಿ**

| ವೇತನ ಶ್ರೇಣಿ ರೂ.5575-10620 | | | | | | | |
|---|---|---|---|---|---|---|---|
| ಕ್ರ. ಸಂ. | ನೌಕರರು ಅಧಿಕಾರಿಯವರ ಹೆಸರು | ನೇರ ನೇಮಕಾತಿ ಮುಂಬಡ್ತಿ/ವರ್ಗಾವಣೆ (ವಿಲೀನತೆ) | ಹುಟ್ಟಿದ ದಿನಾಂಕ | ಸರ್ಕಾರಿ ಸೇವೆಗೆ ಸೇರಿದ ದಿನಾಂಕ | ಪ್ರಸ್ತುತ ಹುದ್ದೆಯಲ್ಲಿ ಅವಿಚ್ಛನ್ನ ಸೇವೆಯ ದಿನಾಂಕ | ನೇಮಕಾತಿಗೆ / ಜೇಷ್ಠತೆಗೆ ಅರ್ಹತಾ ದಿನಾಂಕ | ಷರಾ |
| 1. | ಶ್ರೀ ಎಂ.ಆರ್. ವೆಂಕಟರಂಗಪ್ಪ | ಕೈಗಾರಿಕೆ ಮತ್ತು ವಾಣಿಜ್ಯ ಇಲಾಖೆಯಿಂದ ಕೈಮಗ್ಗ ಮತ್ತು ಜವಳಿ ಇಲಾಖೆಗೆ ವರ್ಗಾವಣೆ (ವಿಲೀನತೆ) ಅಧಿಸೂಚನೆ, ದಿ:26.7.2001. | 13.4.47 | 22.11.72 | 5.1.1994 | 5.1.1994 | ದಿನಾಂಕ 30.4.2005 ರಂದು ವಯೋ ನಿವೃತ್ತಿ ಹೊಂದಿರುತ್ತಾರೆ. |
| 2 | ಶ್ರೀ ಬಿ.ಟಿ. ಪಾಂಡುರಂಗಪ್ಪ | -"- | 2.6.50 | 10.10.72 | 5.1.1994 | 5.1.1994 | ಸದರಿ ಅಧಿಕಾರಿಗಳು ನಿಯಮ 32ರ ಮೇರೆಗೆ ನೇರ ನೇಮಕಾತಿ ಹುದ್ದೆಯ ಕೋಟಾದಲ್ಲಿ ಸಹಾಯಕ ನಿರ್ದೇಶಕರಾಗಿ ಕಾರ್ಯನಿರ್ವಹಿಸುತ್ತಿದ್ದಾರೆ |
| 3 | ಶ್ರೀ ಪಿ.ಡಿ. ಪನ್ನೀರ ಸೆಲ್ವಂ | -"- | 26.5.57 | 16.1.86 | 5.1.1994 | 5.1.1994 | |
| 4 | ಶ್ರೀ ಜಿ.ಪಿ. ಶ್ರೀನಿವಾಸ ಮೂರ್ತಿ | -"- | 28.7.65 | 12.9.88 | 5.1.1994 | 5.1.1994 | |
| 5 | ಶ್ರೀ ಎಸ್. ಜಗದೀಶ್ | ಜವಳಿ ತನಿಖಾಧಿಕಾರಿ ಹುದ್ದೆಯಿಂದ ಬಡ್ತಿ | 10.1.59 | 16.1.86 | 3.1.2003 | 12.9.2001 | ಬಡ್ತಿಗಾಗಿ ರಿಕ್ತಸ್ಥಾನ ಲಭ್ಯವಾದ ದಿನಾಂಕ |
| 6 | ಶ್ರೀ ಜಿ.ಟಿ. ಕುಮಾರ್ | " | 27.7.59 | 16.1.86 | 3.1.2003 | 12.9.2001 | -"- |

**ಕೆ.ಎಲ್. ಜಯರಾಮ್**

ಪಿ.ಆರ್. 1252 ಸರ್ಕಾರದ ಉಪ ಕಾರ್ಯದರ್ಶಿ, ವಾಣಿಜ್ಯ ಮತ್ತು ಕೈಗಾರಿಕೆ ಇಲಾಖೆ.

## ಕಂದಾಯ ಇಲಾಖೆ

**ಅಧಿಸೂಚನೆ ಸಂಖ್ಯೆ:ಕಂಇ 62 ಎಲ್‌ಆರ್‌ಎಂ 2004, ಬೆಂಗಳೂರು, ದಿನಾಂಕ: 29ನೇ ಆಗಸ್ಟ್ 2005**

ದಿ ಕನ್ಸರ್ನ್ಡ್ ಫಾರ್ ವರ್ಕಿಂಗ್ ಚಿಲ್ಡ್ರನ್ ವಿದ್ಯಾ ಸಂಸ್ಥೆ, ಕುಂದಾಪುರ ಇವರು ಬಳ್ಳಾರಿ ಜಿಲ್ಲೆ, ಹಗರಿ ಬೊಮ್ಮನಹಳ್ಳಿ ತಾಲ್ಲೂಕು, ಮೋರಿಗೇರಿ ಗ್ರಾಮದ ಸರ್ವೆ ನಂ. 638 ರಲ್ಲಿ 21 ಎಕರೆ 30 ಗುಂಟೆ ಜಮೀನನ್ನು ಗ್ರಾಮ ಬಾಲ ಕಾರ್ಮಿಕ ವೃತ್ತಿ ತರಬೇತಿ ಕೇಂದ್ರಕ್ಕೆ ಶೈಕ್ಷಣಿಕ ಉದ್ದೇಶಕ್ಕಾಗಿ ಖರೀದಿಸಲು ಮಾಡಿದ ಬೇಡಿಕೆ ಹಾಗೂ ನಮೂನೆ 15-ಎ ಮತ್ತು 15-ಎಎ ಗಳಲ್ಲಿ ನೀಡಿದ ಮಾಹಿತಿ ಅನುಸರಿಸಿ ಜಿಲ್ಲಾಧಿಕಾರಿಗಳು,

ಬಳ್ಳಾರಿ ಜಿಲ್ಲೆ ಇವರು ತಮ್ಮ ಪತ್ರ ಸಂಖ್ಯೆ: ಕಂ/ಭೂಸು/ವಿನಾಯ್ತಿ/1/02-03, ದಿನಾಂಕ: 30.3.2005 ರಲ್ಲಿ ಪ್ರಸ್ತಾಪಿತ ಗ್ರಾಮದ ಸರ್ವೆ ನಂ. 638 ರಲ್ಲಿ 21 ಎಕರೆ 30 ಗುಂಟೆ ಜಮೀನನ್ನು ಖರೀದಿಸಲು ಸದರಿ ಸಂಸ್ಥೆಗೆ ಕರ್ನಾಟಕ ಭೂಸುಧಾರಣೆ ಅಧಿನಿಯಮ, 1961ರ ಕಲಂ 109(1ಎ) ಅಡಿ ವಿನಾಯಿತಿ ನೀಡಲು ಶಿಫಾರಸ್ಸು ಮಾಡಿರುತ್ತಾರೆ.

ಪ್ರಸ್ತಾಪಿತ ಜಮೀನಿನ ಖಾತೆದಾರರಿಂದ ಜಮೀನನ್ನು ಖರೀದಿಸಲು ಕರಾರು ಪತ್ರ ಮಾಡಿಕೊಂಡಿರುತ್ತಾರೆ.

ಪ್ರಸ್ತಾಪಿತ ಜಮೀನು ಕರ್ನಾಟಕ ಪರಿಶಿಷ್ಟ ಜಾತಿ/ಪರಿಶಿಷ್ಟ ಪಂಗಡ (ಪಿ.ಟಿ.ಸಿ.ಎಲ್) ಅಧಿನಿಯಮ, 1978, ಕರ್ನಾಟಕ ಭೂ ಮಂಜೂರಾತಿ ನಿಯಮಾವಳಿಗಳು ಹಾಗೂ ಇನ್ನಿತರ ಪರಭಾರೆ ನಿಷೇಧ ಕಾಯ್ದೆಗಳ ವ್ಯಾಪ್ತಿಗೆ ಒಳಪಡುವುದಿಲ್ಲ.

ರಾಜ್ಯ ಸರ್ಕಾರವು ಸಾರ್ವಜನಿಕ ಹಿತಾಸಕ್ತಿಯ ಮೇರೆಗೆ, ಕಾರಣಗಳನ್ನು ದಾಖಲಿಸಿ ನಿರ್ದಿಷ್ಟ ಉದ್ದೇಶಕ್ಕಾಗಿ ಎಷ್ಟೇ ವಿಸ್ತೀರ್ಣದ ಭೂಮಿಯನ್ನು, ಷರತ್ತು ಮತ್ತು ನಿಬಂಧನೆಗಳನ್ನು ವಿಧಿಸಿ, ಕರ್ನಾಟಕ ಭೂಸುಧಾರಣೆ ಅಧಿನಿಯಮ, 1961ರ ಕಲಂ 63, 79ಎ, 79ಬಿ ಅಥವಾ 80ರ ಅವಕಾಶಗಳಿಂದ ವಿನಾಯಿತಿ ನೀಡಲು ಸದರಿ ಅಧಿನಿಯಮದ ಕಲಂ 109(1ಎ) ರಲ್ಲಿ ಅವಕಾಶ ಕಲ್ಪಿಸಿದೆ.

ಈ ಪ್ರಸ್ತಾವನೆ ಕರ್ನಾಟಕ ಭೂಸುಧಾರಣೆ (ತಿದ್ದುಪಡಿ) ಅಧಿನಿಯಮ, 1995ರ ಕಲಂ 109(1ಎ) ಮತ್ತು ಕರ್ನಾಟಕ ಭೂಸುಧಾರಣೆ (ತಿದ್ದುಪಡಿ) ನಿಯಮಗಳು, 1996ರ ನಿಯಮ 38-ಬಿ ಮತ್ತು 38-ಸಿ ರಲ್ಲಿನ ಷರತ್ತುಗಳನ್ನು ಪೂರೈಸಿದ್ದು, ಕರ್ನಾಟಕ ಭೂಸುಧಾರಣೆ ಅಧಿನಿಯಮ, 1961ರ ಕಲಂ 63, 79ಎ, 79ಬಿ ಅಥವಾ 80ಕ್ಕೆ ವಿನಾಯಿತಿ ನೀಡಿ ದಿ ಕನ್ಸರ್ನ್ಡ್ ಫಾರ್ ವರ್ಕಿಂಗ್ ಚಿಲ್ಡ್ರನ್ ವಿದ್ಯಾ ಸಂಸ್ಥೆ, ಕುಂದಾಪುರ ಇವರು ಬಳ್ಳಾರಿ ಜಿಲ್ಲೆ, ಹಗರಿ ಬೊಮ್ಮನಹಳ್ಳಿ ತಾಲ್ಲೂಕು, ಮೋರಿಗೇರಿ ಗ್ರಾಮದ ಸರ್ವೆ ನಂ. 638 ರಲ್ಲಿ 21 ಎಕರೆ 30 ಗುಂಟೆ ಜಮೀನನ್ನು ಗ್ರಾಮ ಬಾಲ ಕಾರ್ಮಿಕ ವೃತ್ತಿ ತರಬೇತಿ ಕೇಂದ್ರಕ್ಕೆ ಶೈಕ್ಷಣಿಕ ಉದ್ದೇಶಕ್ಕಾಗಿ ಖರೀದಿಸಲು ಕರ್ನಾಟಕ ಭೂಸುಧಾರಣೆ ಅಧಿನಿಯಮ, 1961ರ ಕಲಂ 109(1ಎ) ಅಡಿ ಈ ಕೆಳಕಂಡ ಷರತ್ತುಗಳಿಗೆ ಒಳಪಟ್ಟಂತೆ ಸರ್ಕಾರದ ಅನುಮತಿ ನೀಡಲಾಗಿದೆ.

1. ಯಾವ ಉದ್ದೇಶಕ್ಕಾಗಿ ಜಮೀನನ್ನು ಖರೀದಿಸಲು ಅನುಮತಿ ನೀಡಲಾಗಿದೆಯೋ ಅದೇ ಉದ್ದೇಶಕ್ಕಾಗಿ ಸದರಿ ಜಮೀನನ್ನು ಎರಡು ವರ್ಷಗಳೊಳಗಾಗಿ ಉಪಯೋಗಿಸತಕ್ಕದ್ದು ಮತ್ತು ಆ ಬಗ್ಗೆ ಜಿಲ್ಲಾಧಿಕಾರಿಗಳ ಮುಖಾಂತರ ಸರ್ಕಾರಕ್ಕೆ ಲಿಖಿತವಾಗಿ ಮಾಹಿತಿ ನೀಡತಕ್ಕದ್ದು.
2. ವಿನಾಯಿತಿ ಪಡೆದವರು ಸರ್ಕಾರ ಅಥವಾ ಯಾವುದೇ ಷೆಡ್ಯೂಲ್ ಬ್ಯಾಂಕ್ ಅಥವಾ ಸಹಕಾರಿ, ಕೃಷಿ ಮತ್ತು ಗ್ರಾಮೀಣಾಭಿವೃದ್ಧಿ ಬ್ಯಾಂಕ್ ಒಂದಕ್ಕೆ ಅಥವಾ ಕಂಪನಿ ಕಾಯ್ದೆ, 1956ರ ಕಲಂ 3 ರಲ್ಲಿ ಹೇಳಿರುವಂತೆ ಶೇಕಡ 55 ಪೇಯ್ಡ್ ಅಪ್ ಷೇರು ಬಂಡವಾಳ ಹೊಂದಿದ ರಾಜ್ಯ ಸರ್ಕಾರ ಅಥವಾ ಕೇಂದ್ರ ಸರ್ಕಾರ ಅಥವಾ ರಾಜ್ಯ ಸರ್ಕಾರದ ನಿಯಂತ್ರಿತ ಅಥವಾ ಎರಡರ ಹಿಡಿತ ಹೊಂದಿರುವ ಸರ್ಕಾರದ ಸಂಘ/ಸಂಸ್ಥೆ ಒಂದಕ್ಕೆ ಖಾತರಿ ನೀಡಿ ಅಡಮಾನ ಹಾಗೂ ಇತರೆ ಹೊಣೆ ಮಾಡಿ ಸಾಲ ಪಡೆಯುವುದನ್ನು ಹೊರತುಪಡಿಸಿ ಸದರಿ ಜಮೀನನ್ನು ನಿಗದಿತ ಉದ್ದೇಶಕ್ಕಲ್ಲದೆ ಬೇರೆ ಉದ್ದೇಶಕ್ಕೆ ಬಳಸತಕ್ಕದ್ದಲ್ಲ.
3. ಜಮೀನು ನಗರಾಭಿವೃದ್ಧಿ ಪ್ರಾಧಿಕಾರದ ಸಿ.ಡಿ.ಪಿ/ಒ.ಡಿ.ಪಿ. ವ್ಯಾಪ್ತಿಯೊಳಗೆ ಬಂದರೆ, ಅದರಂತೆ ಅನುಮತಿ ಪಡೆದು ಉಪಯೋಗಿಸತಕ್ಕದ್ದು.
4. ಈ ಅನುಮತಿಯು ಕರ್ನಾಟಕ ಭೂಸುಧಾರಣೆ ಅಧಿನಿಯಮ, 1961ರ ಕಲಂ 109 ರನ್ವಯ ವಿನಾಯಿತಿ ಮಾತ್ರವಾಗಿರುತ್ತದೆ. ಬೇರೆ ಕಾನೂನುಗಳ ಉಲ್ಲಂಘನೆಯಾದಲ್ಲಿ ಸಂಬಂಧಿಸಿದ ಕಾಯ್ದೆಯಡಿ ಅಗತ್ಯ ಕ್ರಮ ಜರುಗಿಸಲು ಅವಕಾಶವಿರುತ್ತದೆ.
5. ಈ ಜಮೀನನ್ನು ವ್ಯವಸಾಯದಿಂದ ವ್ಯವಸಾಯೇತರ ಉದ್ದೇಶಕ್ಕಾಗಿ ಪರಿವರ್ತಿಸಿಕೊಳ್ಳಲು ಕರ್ನಾಟಕ ಭೂ ಕಂದಾಯ ಅಧಿನಿಯಮ, 1964ರ ಕಲಂ 95 ರಂತೆ ಜಿಲ್ಲಾಧಿಕಾರಿಗಳಿಂದ ಅನುಮತಿ ಪಡೆಯತಕ್ಕದ್ದು.
6. ಸಂಸ್ಥೆ ನಡೆಸುವ ಚಟುವಟಿಕೆಗಳು ಸ್ಥಳೀಯ ಕಾನೂನು, ಕರ್ನಾಟಕ ಮತ್ತು ಭಾರತದ ಕಾನೂನುಗಳನ್ನು ಪಾಲಿಸತಕ್ಕದ್ದು.
7. ಪ್ರಸ್ತಾಪಿತ ಜಮೀನುಗಳಲ್ಲಿ ಯಾವುದೇ ಅಭಿವೃದ್ಧಿ ಕಾರ್ಯ ಕೈಗೊಳ್ಳುವ ಮೊದಲು ಜಮೀನಿನ ವಿನ್ಯಾಸಕ್ಕೆ ನಗರ ಯೋಜನಾ ಇಲಾಖೆ/ಅಭಿವೃದ್ಧಿ ಪ್ರಾಧಿಕಾರ ಸ್ಥಳೀಯ ಪ್ರಾಧಿಕಾರಗಳಿಂದ ಅನುಮೋದನೆ ಪಡೆಯತಕ್ಕದ್ದು.
8. ಮೇಲಿನ ಷರತ್ತುಗಳು ಉಲ್ಲಂಘನೆಯಾದಲ್ಲಿ ಈಗ ನೀಡಲಾಗಿರುವ ಅನುಮತಿಯನ್ನು ಕಾನೂನು ರೀತ್ಯ ರದ್ದುಪಡಿಸಲಾಗುವುದು ಮತ್ತು ಪ್ರಸ್ತಾಪಿತ ಭೂಮಿಯನ್ನು ಋಣಮುಕ್ತವಾಗಿ ಸರ್ಕಾರದಲ್ಲಿ ನಿಹಿತ ಮಾಡಿಕೊಳ್ಳಲಾಗುವುದು.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 1253

**ಶಿವಲಿಂಗ**

ಸರ್ಕಾರದ ಅಧೀನ ಕಾರ್ಯದರ್ಶಿ (ಪ್ರ), ಕಂದಾಯ ಇಲಾಖೆ (ಭೂಸುಧಾರಣೆ)

## ಕಂದಾಯ ಇಲಾಖೆ

### ಅಧಿಸೂಚನೆ ಸಂಖ್ಯೆ:ಕಂಇ 60 ಎಲ್‌ಆರ್‌ಎಂ 2005, ಬೆಂಗಳೂರು, ದಿನಾಂಕ: 26ನೇ ಆಗಸ್ಟ್ 2005

ಶ್ರೀ ಜಗದ್ಗುರು ವೀರಗಂಗಾಧರ ಶಿವಾಚಾರ್ಯ ತ್ರಿಕೋಟಿ ಶಿವಲಿಂಗ ಟ್ರಸ್ಟ್, ಮುಕ್ತಿಮಂದಿರ ಇವರು ಧಾರವಾಡ ಜಿಲ್ಲೆ, ಕುಂದಗೋಳ ತಾಲ್ಲೂಕು, ಕಳಸ ಗ್ರಾಮದ ಸರ್ವೆ ನಂ. 101/1ಬಿ/6, 101/1ಬಿ/8ಸಿ, 101/1ಬಿ/7ಎ, 101/1ಬಿ/7ಬಿ, 101/1ಬಿ/7ಸಿ, 101/1ಬಿ/7ಡಿ, 101/1ಬಿ/8ಬಿ, 101/1ಬಿ/10, 101/1ಬಿ/6 ಮತ್ತು 101/1ಡಿ/3ಡಿ, ಒಟ್ಟು 41-00 ಎಕರೆ ಜಮೀನನ್ನು ಮೂರು ಕೋಟಿ ಶಿವಲಿಂಗಗಳನ್ನು ಸ್ಥಾಪಿಸುವ ಉದ್ದೇಶಕ್ಕಾಗಿ ಖರೀದಿಸಲು ಮಾಡಿದ ಬೇಡಿಕೆ ಹಾಗೂ ನಮೂನೆ 15-ಎ ಮತ್ತು 15-ಎಎ ಗಳಲ್ಲಿ ನೀಡಿದ ಮಾಹಿತಿ ಅನುಸರಿಸಿ ಜಿಲ್ಲಾಧಿಕಾರಿಗಳು, ಧಾರವಾಡ ಜಿಲ್ಲೆ ಇವರು ತಮ್ಮ ಪತ್ರ ಸಂಖ್ಯೆ: ಕೆಎಲ್‌ಆರ್/ವಿ/ಸಿಆರ್/03/05-06, ದಿನಾಂಕ: 6.6.2005 ರಲ್ಲಿ ಪ್ರಸ್ತಾಪಿತ ಗ್ರಾಮದ ಮೇಲ್ಕಂಡ ಸರ್ವೆ ನಂಬರುಗಳಲ್ಲಿ ಒಟ್ಟು 41-00 ಎಕರೆ ಜಮೀನನ್ನು ಖರೀದಿಸಲು ಸದರಿ ಸಂಸ್ಥೆಗೆ ಕರ್ನಾಟಕ ಭೂಸುಧಾರಣೆ ಅಧಿನಿಯಮ, 1961ರ ಕಲಂ 109(1ಎ) ಅಡಿ ವಿನಾಯಿತಿ ನೀಡಲು ಶಿಫಾರಸ್ಸು ಮಾಡಿರುತ್ತಾರೆ.

ಪ್ರಸ್ತಾಪಿತ ಜಮೀನಿನ ಖಾತೆದಾರರಿಂದ ಜಮೀನನ್ನು ಖರೀದಿಸಲು ಕರಾರು ಪತ್ರ ಮಾಡಿಕೊಂಡಿರುತ್ತಾರೆ.

ಪ್ರಸ್ತಾಪಿತ ಜಮೀನು ಕರ್ನಾಟಕ ಪರಿಶಿಷ್ಟ ಜಾತಿ/ಪರಿಶಿಷ್ಟ ಪಂಗಡ (ಪಿ.ಟಿ.ಸಿ.ಎಲ್) ಅಧಿನಿಯಮ, 1978, ಕರ್ನಾಟಕ ಭೂ ಮಂಜೂರಾತಿ ನಿಯಮಾವಳಿಗಳು ಹಾಗೂ ಇನ್ನಿತರ ಪರಭಾರೆ ನಿಷೇಧ ಕಾಯ್ದೆಗಳ ವ್ಯಾಪ್ತಿಗೆ ಒಳಪಡುವುದಿಲ್ಲ.

ರಾಜ್ಯ ಸರ್ಕಾರವು ಸಾರ್ವಜನಿಕ ಹಿತಾಸಕ್ತಿಯ ಮೇರೆಗೆ, ಕಾರಣಗಳನ್ನು ದಾಖಲಿಸಿ ನಿರ್ದಿಷ್ಟ ಉದ್ದೇಶಕ್ಕಾಗಿ ಎಷ್ಟೇ ವಿಸ್ತೀರ್ಣದ ಭೂಮಿಯನ್ನು, ಷರತ್ತು ಮತ್ತು ನಿಬಂಧನೆಗಳನ್ನು ವಿಧಿಸಿ, ಕರ್ನಾಟಕ ಭೂಸುಧಾರಣೆ ಅಧಿನಿಯಮ, 1961ರ ಕಲಂ 63, 79ಎ, 79ಬಿ ಅಥವಾ 80ರ ಅವಕಾಶಗಳಿಂದ ವಿನಾಯಿತಿ ನೀಡಲು ಸದರಿ ಅಧಿನಿಯಮದ ಕಲಂ 109(1ಎ) ರಲ್ಲಿ ಅವಕಾಶ ಕಲ್ಪಿಸಿದೆ.

ಈ ಪ್ರಸ್ತಾವನೆ ಕರ್ನಾಟಕ ಭೂಸುಧಾರಣೆ (ತಿದ್ದುಪಡಿ) ಅಧಿನಿಯಮ, 1995ರ ಕಲಂ 109(1ಎ) ಮತ್ತು ಕರ್ನಾಟಕ ಭೂಸುಧಾರಣೆ (ತಿದ್ದುಪಡಿ) ನಿಯಮಗಳು, 1996ರ ನಿಯಮ 38-ಬಿ ಮತ್ತು 38-ಸಿ ರಲ್ಲಿನ ಷರತ್ತುಗಳನ್ನು ಪೂರೈಸಿದ್ದು, ಕರ್ನಾಟಕ ಭೂಸುಧಾರಣೆ ಅಧಿನಿಯಮ, 1961ರ ಕಲಂ 63, 79ಎ, 79ಬಿ ಅಥವಾ 80ಕ್ಕೆ ವಿನಾಯಿತಿ ನೀಡಿ ಶ್ರೀ ಜಗದ್ಗುರು ವೀರಗಂಗಾಧರ ಶಿವಾಚಾರ್ಯ ತ್ರಿಕೋಟಿ ಶಿವಲಿಂಗ ಟ್ರಸ್ಟ್, ಮುಕ್ತಿಮಂದಿರ ಇವರು ಧಾರವಾಡ ಜಿಲ್ಲೆ, ಕುಂದಗೋಳ ತಾಲ್ಲೂಕು, ಕಳಸ ಗ್ರಾಮದ ಸರ್ವೆ ನಂ. 101/1ಬಿ/6, 101/1ಬಿ/8ಸಿ, 101/1ಬಿ/7ಎ, 101/1ಬಿ/7ಬಿ, 101/1ಬಿ/7ಸಿ, 101/1ಬಿ/7ಡಿ, 101/1ಬಿ/8ಬಿ, 101/1ಬಿ/10, 101/1ಬಿ/6 ಮತ್ತು 101/1ಡಿ/3ಡಿ, ಒಟ್ಟು 41-00 ಎಕರೆ ಜಮೀನನ್ನು ಮೂರು ಕೋಟಿ ಶಿವಲಿಂಗಗಳನ್ನು ಸ್ಥಾಪಿಸುವ ಉದ್ದೇಶಕ್ಕಾಗಿ ಖರೀದಿಸಲು ಕರ್ನಾಟಕ ಭೂಸುಧಾರಣೆ ಅಧಿನಿಯಮ, 1961ರ ಕಲಂ 109(1ಎ) ಅಡಿ ಈ ಕೆಳಕಂಡ ಷರತ್ತುಗಳಿಗೆ ಒಳಪಟ್ಟಂತೆ ಸರ್ಕಾರದ ಅನುಮತಿ ನೀಡಲಾಗಿದೆ.

1. ಯಾವ ಉದ್ದೇಶಕ್ಕಾಗಿ ಜಮೀನನ್ನು ಖರೀದಿಸಲು ಅನುಮತಿ ನೀಡಲಾಗಿದೆಯೋ ಅದೇ ಉದ್ದೇಶಕ್ಕಾಗಿ ಸದರಿ ಜಮೀನನ್ನು ಎರಡು ವರ್ಷಗಳೊಳಗಾಗಿ ಉಪಯೋಗಿಸತಕ್ಕದ್ದು ಮತ್ತು ಆ ಬಗ್ಗೆ ಜಿಲ್ಲಾಧಿಕಾರಿಗಳ ಮುಖಾಂತರ ಸರ್ಕಾರಕ್ಕೆ ಲಿಖಿತವಾಗಿ ಮಾಹಿತಿ ನೀಡತಕ್ಕದ್ದು.
2. ವಿನಾಯಿತಿ ಪಡೆದವರು ಸರ್ಕಾರ ಅಥವಾ ಯಾವುದೇ ಷೆಡ್ಯೂಲ್ ಬ್ಯಾಂಕ್ ಅಥವಾ ಸಹಕಾರಿ, ಕೃಷಿ ಮತ್ತು ಗ್ರಾಮೀಣಾಭಿವೃದ್ಧಿ ಬ್ಯಾಂಕ್ ಒಂದಕ್ಕೆ ಅಥವಾ ಕಂಪನಿ ಕಾಯ್ದೆ, 1956ರ ಕಲಂ 3 ರಲ್ಲಿ ಹೇಳಿರುವಂತೆ ಶೇಕಡ 55 ಪೇಯ್ಡ್ ಅಪ್ ಷೇರು ಬಂಡವಾಳ ಹೊಂದಿದ ರಾಜ್ಯ ಸರ್ಕಾರ ಅಥವಾ ಕೇಂದ್ರ ಸರ್ಕಾರ ಅಥವಾ ರಾಜ್ಯ ಸರ್ಕಾರದ ನಿಯಂತ್ರಿತ ಅಥವಾ ಎರಡರ ಹಿಡಿತ ಹೊಂದಿರುವ ಸರ್ಕಾರದ ಸಂಘ/ಸಂಸ್ಥೆ ಒಂದಕ್ಕೆ ಖಾತರಿ ನೀಡಿ ಅಡಮಾನ ಹಾಗೂ ಇತರೆ ಹೊಣೆ ಮಾಡಿ ಸಾಲ ಪಡೆಯುವುದನ್ನು ಹೊರತುಪಡಿಸಿ ಸದರಿ ಜಮೀನನ್ನು ನಿಗದಿತ ಉದ್ದೇಶಕ್ಕಲ್ಲದೆ ಬೇರೆ ಉದ್ದೇಶಕ್ಕೆ ಬಳಸತಕ್ಕದ್ದಲ್ಲ.
3. ಜಮೀನು ನಗರಾಭಿವೃದ್ಧಿ ಪ್ರಾಧಿಕಾರದ ಸಿ.ಡಿ.ಪಿ/ಒ.ಡಿ.ಪಿ. ವ್ಯಾಪ್ತಿಯೊಳಗೆ ಬಂದರೆ, ಅದರಂತೆ ಅನುಮತಿ ಪಡೆದು ಉಪಯೋಗಿಸತಕ್ಕದ್ದು.
4. ಈ ಅನುಮತಿಯು ಕರ್ನಾಟಕ ಭೂಸುಧಾರಣೆ ಅಧಿನಿಯಮ, 1961ರ ಕಲಂ 109 ರನ್ವಯ ವಿನಾಯಿತಿ ಮಾತ್ರವಾಗಿರುತ್ತದೆ. ಬೇರೆ ಕಾನೂನುಗಳ ಉಲ್ಲಂಘನೆಯಾದಲ್ಲಿ ಸಂಬಂಧಿಸಿದ ಕಾಯ್ದೆಯಡಿ ಅಗತ್ಯ ಕ್ರಮ ಜರುಗಿಸಲು ಅವಕಾಶವಿರುತ್ತದೆ.
5. ಈ ಜಮೀನನ್ನು ವ್ಯವಸಾಯದಿಂದ ವ್ಯವಸಾಯೇತರ ಉದ್ದೇಶಕ್ಕಾಗಿ ಪರಿವರ್ತಿಸಿಕೊಳ್ಳಲು ಕರ್ನಾಟಕ ಭೂ ಕಂದಾಯ ಅಧಿನಿಯಮ, 1964ರ ಕಲಂ 95 ರಂತೆ ಜಿಲ್ಲಾಧಿಕಾರಿಗಳಿಂದ ಅನುಮತಿ ಪಡೆಯತಕ್ಕದ್ದು.
6. ಸಂಸ್ಥೆ ನಡೆಸುವ ಚಟುವಟಿಕೆಗಳು ಸ್ಥಳೀಯ ಕಾನೂನು, ಕರ್ನಾಟಕ ಮತ್ತು ಭಾರತದ ಕಾನೂನುಗಳನ್ನು ಪಾಲಿಸತಕ್ಕದ್ದು.
7. ಪ್ರಸ್ತಾಪಿತ ಜಮೀನುಗಳಲ್ಲಿ ಯಾವುದೇ ಅಭಿವೃದ್ಧಿ ಕಾರ್ಯ ಕೈಗೊಳ್ಳುವ ಮೊದಲು ಜಮೀನಿನ ವಿನ್ಯಾಸಕ್ಕೆ ನಗರ ಯೋಜನಾ ಇಲಾಖೆ/ಅಭಿವೃದ್ಧಿ ಪ್ರಾಧಿಕಾರ ಸ್ಥಳೀಯ ಪ್ರಾಧಿಕಾರಗಳಿಂದ ಅನುಮೋದನೆ ಪಡೆಯತಕ್ಕದ್ದು.
8. ಮೇಲಿನ ಷರತ್ತುಗಳು ಉಲ್ಲಂಘನೆಯಾದಲ್ಲಿ ಈಗ ನೀಡಲಾಗಿರುವ ಅನುಮತಿಯನ್ನು ಕಾನೂನು ರೀತ್ಯ ರದ್ದುಪಡಿಸಲಾಗುವುದು ಮತ್ತು ಪ್ರಸ್ತಾಪಿತ ಭೂಮಿಯನ್ನು ಋಣಮುಕ್ತವಾಗಿ ಸರ್ಕಾರದಲ್ಲಿ ನಿಹಿತ ಮಾಡಿಕೊಳ್ಳಲಾಗುವುದು.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 1254

**ಶಿವಲಿಂಗ**

ಸರ್ಕಾರದ ಅಧೀನ ಕಾರ್ಯದರ್ಶಿ (ಪ್ರ), ಕಂದಾಯ ಇಲಾಖೆ (ಭೂಸುಧಾರಣೆ)

## ರೇಷ್ಮೆ ಕೃಷಿ ಅಭಿವೃದ್ಧಿ ಆಯುಕ್ತರು ಹಾಗೂ ರೇಷ್ಮೆ ನಿರ್ದೇಶಕರು, ಬೆಂಗಳೂರು ಇವರ ನಡವಳಿಕೆಗಳು

**ವಿಷಯ:** ಶ್ರೀ ಕೆ. ಪ್ರಭುದೇವ, ಪ್ರಥಮ ದರ್ಜೆ ಸಹಾಯಕರು, ಕೇಂದ್ರ ಕಛೇರಿ, ಬೆಂಗಳೂರು ಇವರ ವಿರುದ್ಧ ಶಿಸ್ತು ಕ್ರಮದ ಕುರಿತು.

**ಉಲ್ಲೇಖ:**
1. ಈ ಕಛೇರಿಯ ತಿಳುವಳಿಕೆ ಪತ್ರದ ಸಂಖ್ಯೆ:ಸಿ3-ಶಿಸ್ತು-ಲಿಪಿಕ-01:2004-05 ದಿನಾಂಕ: 16.6.2004.
2. ಆದೇಶ ಸಂಖ್ಯೆ:ಸಿ3:ಶಿಸ್ತು:ಲಿಪಿಕ-01:04-05 ದಿನಾಂಕ: 3.8.2004.
3. ರೇಷ್ಮೆ ಉಪನಿರ್ದೇಶಕರು, ನಿರ್ದೇಶನಾಲಯ, ಬೆಂಗಳೂರು ಇವರ ಪತ್ರದ ಸಂ.ಉನಿ.ಎನ್‌ಪಿಎಸ್‌ಎಫ್:ಇವಿ:02: 04-05 ದಿನಾಂಕ: 2.4.2005.
4. ತಿಳುವಳಿಕೆ ಪತ್ರದ ಸಂ.ಸಿ3:ಶಿಸ್ತು:ಲಿಪಿಕ-01:04-05 ದಿನಾಂಕ:29.4.2005.

**ಪೀಠಿಕೆ:**

ಶ್ರೀ ಕೆ. ಪ್ರಭುದೇವ, ಪ್ರಥಮ ದರ್ಜೆ ಸಹಾಯಕ, ರೇಷ್ಮೆ ನಿರ್ದೇಶನಾಲಯ, ಬೆಂಗಳೂರು ಇವರ ಸೇವೆಯನ್ನು ದಿನಾಂಕ: 22.6.2002ರ ಆದೇಶದಲ್ಲಿ ಶ್ರೀ ಎಂ. ಚಂದ್ರಪ್ಪ , ಶಾಸಕರು ಭರಮಸಾಗರ ಕ್ಷೇತ್ರ, ಚಿತ್ರದುರ್ಗ ಜಿಲ್ಲೆ ಇವರ ಆಪ್ತ ಕಾರ್ಯದರ್ಶಿ ಹುದ್ದೆಗೆ ನಿಯೋಜಿಸಿ ದಿನಾಂಕ 24.6.2002 ರಂದು ರೇಷ್ಮೆ ನಿರ್ದೇಶನಾಲಯದಿಂದ ಬಿಡುಗಡೆಗೊಳಿಸಲಾಗಿತ್ತು. ಇವರು ದಿನಾಂಕ: 24.6.2002 ರಂದು ನಿರ್ದೇಶನಾಲಯದಿಂದ ಕಾರ್ಯ ವಿಮುಕ್ತಿಗೊಂಡು ದಿನಾಂಕ 25.6.2002 ರಂದು ನಿಯೋಜಿಸಿದ ಜಾಗದಲ್ಲಿ ಕಾರ್ಯವರದಿ ಮಾಡಿಕೊಂಡಿರುತ್ತಾರೆ. ದಿನಾಂಕ 21.7.2003 ರಂದು ಶ್ರೀ ಎಂ. ಚಂದ್ರಪ್ಪ, ಶಾಸಕರು, ಭರಮಸಾಗರ, ಚಿತ್ರದುರ್ಗ ಜಿಲ್ಲೆ ಇವರು ಸರಕಾರಕ್ಕೆ ವರದಿ ಸಲ್ಲಿಸಿ, ಶ್ರೀ ಕೆ. ಪ್ರಭುದೇವ, ಪ್ರಥಮ ದರ್ಜೆ ಸಹಾಯಕ ಇವರು ಜನವರಿ 2003 ರಿಂದ ಗೈರು ಹಾಜರಿಯಾಗಿರುವುದರಿಂದ ಇವರ ಸೇವೆಯನ್ನು ವಾಪಸ್ಸು ಪಡೆಯಲು ಕೋರಿರುತ್ತಾರೆ. ಈ ಹಿನ್ನೆಲೆಯಲ್ಲಿ ಜಿಲ್ಲಾಧಿಕಾರಿಗಳು, ಚಿತ್ರದುರ್ಗ ಜಿಲ್ಲೆ ಇವರು ದಿನಾಂಕ: 7.10.2003ರ ಆದೇಶದಲ್ಲಿ ಶ್ರೀ ಕೆ. ಪ್ರಭುದೇವ, ಪ್ರಥಮ ದರ್ಜೆ ಸಹಾಯಕ ಇವರನ್ನು ಆಪ್ತ ಸಹಾಯಕರ ಹುದ್ದೆಯಿಂದ ಬಿಡುಗಡೆಗೊಳಿಸಿ ರೇಷ್ಮೆ ಇಲಾಖೆಗೆ ವಾಪಸ್ಸು ನೀಡಿರುತ್ತಾರೆ. ಆದರೆ ಶ್ರೀ ಕೆ. ಪ್ರಭುದೇವ, ಪ್ರಥಮ ದರ್ಜೆ ಸಹಾಯಕ ಇವರು ರೇಷ್ಮೆ ನಿರ್ದೇಶನಾಲಯದಲ್ಲಿ ಕಾರ್ಯವರದಿ ಮಾಡಿಕೊಳ್ಳದೆ ಅನಧಿಕೃತವಾಗಿ ಗೈರು ಹಾಜರಾಗಿರುತ್ತಾರೆ. ಶ್ರೀ ಕೆ. ಪ್ರಭುದೇವ ರವರಿಗೆ ಕೆಲಸಕ್ಕೆ ಹಾಜರಾಗುವಂತೆ ನಿರ್ದೇಶನಾಲಯದಿಂದ ದಿನಾಂಕ 6.3.2004, 5.4.2004 ರಂದು ಜ್ಞಾಪನವನ್ನು ಇವರ ನಿವಾಸದ ವಿಳಾಸಕ್ಕೆ ರವಾನಿಸಿದ್ದರೂ ಶ್ರೀ ಕೆ. ಪ್ರಭುದೇವ ರವರು ಯಾವುದೇ ಪ್ರತಿಕ್ರಿಯೆ ವ್ಯಕ್ತಪಡಿಸಿರುವುದಿಲ್ಲ. ಶ್ರೀ ಕೆ. ಪ್ರಭುದೇವರವರು ಅನಧಿಕೃತವಾಗಿ ಗೈರು ಹಾಜರಿಯಲ್ಲಿಯೇ

ಮುಂದುವರಿಯುತ್ತಿದ್ದುದರಿಂದ ಇವರ ವಿರುದ್ಧ ಶಿಸ್ತು ಕ್ರಮ ಜರುಗಿಸಲು ಸಿ.ಸಿ.ಎ. ನಿಯಮ 11 ರಡಿಯಲ್ಲಿ ದಿನಾಂಕ 16.6.2004 ರಂದು ಆರೋಪ ಪಟ್ಟಿಯನ್ನು ತಿಳುವಳಿಕೆ ಪತ್ರದೊಂದಿಗೆ ಜಾರಿಗೊಳಿಸಲಾಯಿತು. ಈ ತಿಳುವಳಿಕೆ ಪತ್ರಕ್ಕೆ ಇವರು ಯಾವುದೇ ರೀತಿಯ ಹೇಳಿಕೆ ನೀಡದೆ ಅನಧಿಕೃತ ಗೈರು ಹಾಜರಿಯನ್ನು ಮುಂದುವರಿಸಿಕೊಂಡು ಹೋಗಿರುತ್ತಾರೆ. ಇದರಿಂದ ಆರೋಪದ ಸತ್ಯಾಸತ್ಯತೆಯನ್ನು ಕಂಡು ಹಿಡಿಯಲು ವಿಚಾರಣೆ ನಡೆಸುವುದು ಅನಿವಾರ್ಯವಾದ್ದರಿಂದ ದಿನಾಂಕ: 3.8.2004 ಆದೇಶದಲ್ಲಿ ವಿಚಾರಣಾಧಿಕಾರಿ ಮತ್ತು ಮಂಡನಾಧಿಕಾರಿಯವರನ್ನು ನೇಮಿಸಿ ವಿಚಾರಣೆ ನಡೆಸಲು ಆದೇಶಿಸಲಾಯಿತು. ವಿಚಾರಣಾಧಿಕಾರಿಗಳು ಸಿ.ಸಿ.ಎ. ನಿಯಮ 11 ರಡಿಯಲ್ಲಿ ನಿರ್ದಿಷ್ಟಪಡಿಸಿರುವ ವಿಧಿ ವಿಧಾನಗಳನ್ನು ಅನುಸರಿಸಿ ವಿಚಾರಣೆ ನಡೆಸಿ ದಿನಾಂಕ 2.4.2005 ರಂದು ಶಿಸ್ತು ಪ್ರಾಧಿಕಾರಕ್ಕೆ ವಿಚಾರಣಾ ವರದಿಯನ್ನು ದಾಖಲೆಗಳೊಂದಿಗೆ ಸಲ್ಲಿಸಿರುತ್ತಾರೆ. ವಿಚಾರಣಾ ವರದಿಯನ್ನು ಪರಿಶೀಲಿಸಲಾಗಿ, ಈ ಇಲಾಖಾ ವಿಚಾರಣೆಗೂ ಶ್ರೀ ಕೆ. ಪ್ರಭುದೇವ, ಪ್ರಥಮ ದರ್ಜೆ ಸಹಾಯಕ ಹಾಜರಾಗುವುದಿಲ್ಲ. ವಿಚಾರಣೆಗೆ ಹಾಜರಾಗಲು ಸೂಚಿಸಿ ವಿಚಾರಣಾಧಿಕಾರಿಗಳು ರವಾನಿಸಿರುವ ಸೂಚನಾ ಪತ್ರಗಳು ಇವರು ವಾಸಸ್ಥಳದಲ್ಲಿ ವಾಸಿಸುತ್ತಿಲ್ಲದ್ದರಿಂದ ಅಂಚೆ ಇಲಾಖೆಯಿಂದ ವಾಪಸ್ಸು ಬಂದಿರುತ್ತದೆ. ಇದರಿಂದ ವಿಚಾರಣಾಧಿಕಾರಿಗಳು ಇವರ ಅನುಪಸ್ಥಿತಿಯಲ್ಲಿ ವಿಚಾರಣೆಯನ್ನು ಸಿ.ಸಿ.ಎ. ನಿಯಮ 11(20) ರಲ್ಲಿ ನಿರ್ದಿಷ್ಟಪಡಿಸಿರುವ ನಿಯಮ ಅನುಸರಿಸಿ ವಿಚಾರಣೆ ನಡೆಸಿರುತ್ತಾರೆ. ವಿಚಾರಣೆಯಲ್ಲಿ ಇವರ ವಿರುದ್ಧ ಮಾಡಲಾದ ಆರೋಪವು ದಾಖಲೆ ಹಾಗೂ ಸಾಕ್ಷಿಗಳ ಹೇಳಿಕೆಯಿಂದ ಸಾಬೀತಾಗಿರುತ್ತದೆ. ವಿಚಾರಣಾಧಿಕಾರಿಗಳ ನಿರ್ಣಯದ ಬಗ್ಗೆ ಲಿಖಿತ ಹೇಳಿಕೆ ಸಲ್ಲಿಸುವಂತೆ ಸೂಚಿಸಿ, ವಿಚಾರಣಾ ವರದಿಯನ್ನು ಶ್ರೀ ಕೆ. ಪ್ರಭುದೇವ, ಪ್ರಥಮ ದರ್ಜೆ ಸಹಾಯಕ ಇವರ ನಿವಾಸದ ವಿಳಾಸಕ್ಕೆ ನೊಂದಾಯಿತ ಅಂಚೆ ಮೂಲಕ ರವಾನಿಸಲಾಯಿತು. ಆದರೆ ಈ ವರದಿಯೂ ಸಹ ಜಾರಿಯಾಗದೆ ಅಂಚೆ ಇಲಾಖೆಯಿಂದ ವಾಪಸ್ಸು ಬಂದಿರುತ್ತದೆ. ಪತ್ರ ವ್ಯವಹಾರದಲ್ಲಿ ಶ್ರೀ ಕೆ. ಪ್ರಭುದೇವ, ಪ್ರಥಮ ದರ್ಜೆ ಸಹಾಯಕ ಇವರನ್ನು ಸಂಪರ್ಕಿಸಲು ನಡೆಸಿರುವ ಪ್ರಯತ್ನಗಳು ವಿಫಲವಾಗಿರುವುದರಿಂದ ಸಿ.ಸಿ.ಎ. ನಿಯಮ 28(ಎ) ರಂತೆ 'ಪ್ರಜಾವಾಣಿ' ಮತ್ತು 'ವಿಜಯ ಕರ್ನಾಟಕ' ದೈನಂದಿನ ವೃತ್ತ ಪತ್ರಿಕೆಯಲ್ಲಿ ದಿನಾಂಕ 27.7.2005 ರಂದು ಪ್ರಕಟಣೆ ಹೊರಡಿಸಿ ಕೆಲಸಕ್ಕೆ ಹಾಜರಾಗಲು ಸೂಚಿಸಿ 15 ದಿನ ಕಾಲಾವಕಾಶ ನೀಡಿದರೂ ಶ್ರೀ ಕೆ. ಪ್ರಭುದೇವರವರು ಯಾವುದೇ ರೀತಿಯಲ್ಲಿ ಸ್ಪಂದಿಸಿರುವುದಿಲ್ಲ.

ಮೇಲಿನ ವಾಸ್ತವಾಂಶವನ್ನು ಗಮನಿಸಿದಾಗ ಶ್ರೀ ಕೆ. ಪ್ರಭುದೇವ, ಪ್ರಥಮ ದರ್ಜೆ ಸಹಾಯಕ, ರೇಷ್ಮೆ ನಿರ್ದೇಶನಾಲಯ, ಬೆಂಗಳೂರು ಇವರು ದಿನಾಂಕ: 1.2.2003 ರಿಂದ ಕಛೇರಿ ಕೆಲಸಕ್ಕೆ ಅನಧಿಕೃತವಾಗಿ ಗೈರು ಹಾಜರಿಯಾಗುತ್ತಿರುವುದು ದಾಖಲೆಯಿಂದ ದೃಢಪಡುತ್ತದೆ. ಕೆಲಸಕ್ಕೆ ಹಾಜರಾಗುವಂತೆ ಸೂಚಿಸಿರುವ ಪತ್ರಕ್ಕೂ ಇವರು ಯಾವುದೇ ರೀತಿಯಲ್ಲೂ ಸ್ಪಂದಿಸಿರುವುದಿಲ್ಲ. ಈ ಹಂತದಲ್ಲಿ ಸಿ.ಸಿ.ಎ. ನಿಯಮದಡಿಯಲ್ಲಿ ನಡೆಸಲಾದ ಇಲಾಖಾ ವಿಚಾರಣೆಗೂ ಇವರು ಗೈರು ಹಾಜರಿಯಾಗಿರುವುದು ಪ್ರದರ್ಶಿತ ದಾಖಲೆಯಿಂದ ದೃಢಪಡುತ್ತದೆ. ಇದರಿಂದ ವಿಚಾರಣೆಯನ್ನು ಸಿ.ಸಿ.ಎ. ನಿಯಮ 11(20) ರಂತೆ ನಡೆಸಲಾಗಿದೆ. ವಿಚಾರಣೆಯಲ್ಲಿ ಪರೀಕ್ಷಿಸಲ್ಪಟ್ಟ ದಾಖಲೆ, ವಿಚಾರಣೆಯಲ್ಲಿ ಸಾಕ್ಷಿಗಳು ನೀಡಿರುವ ಹೇಳಿಕೆ ಎಲ್ಲವೂ ಇವರ ಗೈರು ಹಾಜರಿಯನ್ನು ಸಾಬೀತುಪಡಿಸುತ್ತದೆ. ವಿಚಾರಣಾ ವರದಿಯ ಪ್ರತಿಯನ್ನು ಇವರ ನಿವಾಸದ ವಿಳಾಸಕ್ಕೆ ಕಳುಹಿಸಲಾಗಿದ್ದರೂ ಅದನ್ನು ಸಹ ಪಡೆಯದೇ ಕರ್ತವ್ಯ ಲೋಪವೆಸಗಿರುತ್ತಾರೆ. ಅಂತಿಮವಾಗಿ ಇವರನ್ನು ಸಂಪರ್ಕಿಸಲು ದೈನಂದಿನ ವೃತ್ತ ಪತ್ರಿಕೆಯಲ್ಲಿ ಪ್ರಕಟಿಸಲಾದ ಜಾಹೀರಾತು ಕೂಡ ಇವರು ಗೈರು ಹಾಜರಿಗೆ ಸಾಕ್ಷಿಯಾಗಿರುತ್ತದೆ. ಇವುಗಳೆಲ್ಲವನ್ನು ಗಮನಿಸಿದಾಗ ಶ್ರೀ ಕೆ. ಪ್ರಭುದೇವ, ಪ್ರಥಮ ದರ್ಜೆ ಸಹಾಯಕ ಇವರಿಗೆ ಸರಕಾರಿ ಕೆಲಸದಲ್ಲಿ ಯಾವುದೇ ಆಸಕ್ತಿ ಇಲ್ಲದಿರುವುದು ದೃಢಪಡುತ್ತದೆ. ಒಬ್ಬ ಜವಾಬ್ದಾರಿಯುತ ಸರಕಾರಿ ನೌಕರನಾದ ಶ್ರೀ ಕೆ. ಪ್ರಭುದೇವ, ರವರು ಸರಕಾರಿ ಕೆಲಸದಲ್ಲಿ ತೋರಬೇಕಾದ ಕನಿಷ್ಠ ನಿಷ್ಠೆಯನ್ನು ತೋರದಿರುವುದು ವ್ಯಕ್ತವಾಗುತ್ತದೆ. ವಿಚಾರಣೆಯಲ್ಲಿ ಒದಗಿಸಿರುವ ಸಾಕ್ಷಿ, ಆರೋಪ ಪರ ಪ್ರದರ್ಶಿತ ದಾಖಲೆಗಳನ್ನು ಪರಾಮರ್ಶಿಸಿದಾಗ ಆಪಾದಿತರ ವಿರುದ್ಧ ಮಾಡಲಾದ ಆರೋಪವು ಸಾಬೀತಾಗಿರುವುದರಿಂದ ಇವರಿಗೆ ದಂಡನೆ ವಿಧಿಸಲು ಈ ಆದೇಶ.

**ಆದೇಶ ಸಂಖ್ಯೆ:ಸಿ3:ಶಿಸ್ತು:ಲಿಪಿಕ-01:2004-2005, ದಿನಾಂಕ: 30ನೇ ಆಗಸ್ಟ್ 2005**

ಪೀಠಿಕೆಯಲ್ಲಿ ವಿವರಿಸಿರುವ ಅಂಶಗಳನ್ವಯ ಹಾಗೂ 1957 ಕರ್ನಾಟಕ ಸರ್ಕಾರಿ ಸೇವಾ (ವರ್ಗೀಕರಣ, ನಿಯಂತ್ರಣ ಮತ್ತು ಮೇಲ್ಮನವಿ) ನಿಯಮ 9ನೇ ಅಡಿಯಲ್ಲಿ ಪ್ರದತ್ತವಾದ ಅಧಿಕಾರವನ್ನು ಚಲಾಯಿಸುತ್ತಾ, ಅರವಿಂದ ಜನ್ನು, ರೇಷ್ಮೆ ಕೃಷಿ ಅಭಿವೃದ್ಧಿ ಆಯುಕ್ತರು ಹಾಗೂ ರೇಷ್ಮೆ ನಿರ್ದೇಶಕರು:ಶಿಸ್ತು ಪ್ರಾಧಿಕಾರಿಯಾದ ನಾನು ಶ್ರೀ ಕೆ. ಪ್ರಭುದೇವ, ಪ್ರಥಮ ದರ್ಜೆ ಸಹಾಯಕ, ಕೇಂದ್ರ ಕಛೇರಿ, ಬೆಂಗಳೂರು ಇವರನ್ನು ಈ ತಕ್ಷಣದಿಂದ ಜಾರಿಗೆ ಬರುವಂತೆ ಕೆ.ಸಿ.ಎಸ್. (ಸಿ.ಸಿ.ಎ) ನಿಯಮ 8 (viii)ರಲ್ಲಿ ನಿರ್ದಿಷ್ಟಪಡಿಸಿರುವಂತೆ ಸೇವೆಯಿಂದ ವಜಾ ಮಾಡಿರುತ್ತೇನೆ.

ಪಿ.ಆರ್. 1255 ರೇಷ್ಮೆ ಕೃಷಿ ಅಭಿವೃದ್ಧಿ ಆಯುಕ್ತರು ಹಾಗೂ ರೇಷ್ಮೆ ನಿರ್ದೇಶಕರು, ಶಿಸ್ತು ಪ್ರಾಧಿಕಾರಿಗಳು.

## ಅಧಿಕೃತ ಅಧಿಕಾರಿಗಳು ಹಾಗೂ ಅಬಕಾರಿ ಅಧೀಕ್ಷಕರು, ಇ.ಐ.ಬಿ. ಕೊಡಗು ಜಿಲ್ಲೆ, ಮಡಿಕೇರಿ ರವರ ನಡವಳಿಕೆಗಳು

**ಸಂ:ಇಎಕ್ಸ್‌ಇ:3:ಡಿಟಿಸಿಆರ್‌ಎಂ:185/2003-04, ದಿನಾಂಕ: 10ನೇ ಆಗಸ್ಟ್ 2005**

**ಉಪಸ್ಥಿತರು:** ಶ್ರೀ ಎನ್.ಎಂ. ಹುಸೇನ್,
ಅಧಿಕೃತ ಅಧಿಕಾರಿ ಹಾಗೂ ಅಬಕಾರಿ ಅಧೀಕ್ಷಕರು, ಇ.ಐ.ಬಿ.
ಕೊಡಗು ಜಿಲ್ಲೆ, ಮಡಿಕೇರಿ.

| **ಫಿರ್ಯಾದುದಾರರು** | **ವಿರುದ್ಧ** | **ಅಪರಾಧಿಗಳು** |
|---|---|---|
| ಅಬಕಾರಿ ಉಪ ನಿರೀಕ್ಷಕರು<br>ಉಪ ವಿಭಾಗ, ಮಡಿಕೇರಿ. | | 1. ಟಿ.ಪಿ. ಸಜೀವ (ವಾಹನ ಚಾಲಕ) ತಂದೆ ತಂಗಚ್ಚನ್,<br>ತಚ್ಚಂವಳ್ಳೀ ಹೌಸ್, ವೆಸ್ಟ್ ಎಳೆರಿ ಗ್ರಾಮ, ಬಮನಡಿ ಅಂಚೆ,<br>ಹೊಸದುರ್ಗ, ಕಾನಂಗಾಡ್, ಕಾಸರಗೋಡು ಜಿಲ್ಲೆ.<br>ಮತ್ತು ಇತರರು.<br>2. ಶ್ರೀಮತಿ ಎಂ.ಜಿ. ನಿಲಾಂಬಿಕ, ಗಂಡ ಗುರುಸ್ವಾಮಿ,<br>ನಂ:559, ಇ ಬ್ಲಾಕ್ 3ನೇ ಕ್ರಾಸ್, ಜೆ.ಪಿ. ನಗರ,<br>ಮೈಸೂರು, ವಾಹನದ ಮಾಲೀಕರು. |

**ಪ್ರಕರಣದ ಮುಖ್ಯಾಂಶಗಳು:**

ದಿನಾಂಕ: 25.2.2004 ರಂದು ಮಡಿಕೇರಿ ಉಪ ವಿಭಾಗದ ಉಪ ನಿರೀಕ್ಷಕರು ತಮ್ಮ ಸಿಬ್ಬಂದಿಯ ಜೊತೆ ಮಡಿಕೇರಿ ಸರಹದ್ದಿನಲ್ಲಿ ಗಸ್ತು ತಿರುಗುತ್ತಿದ್ದಾಗ ದೊರೆತ ಖಚಿತ ವರ್ತಮಾನದ ಮೇರೆಗೆ ಮಡಿಕೇರಿಯ ವಿದ್ಯಾನಗರದ ಆರೋಪಿಯ ಮನೆಯಲ್ಲಿ ಶೋಧಿಸಲಾಗಿ ಮನೆಯಲ್ಲಿ ಅಕ್ರಮವಾಗಿ 315 ಲೀ, ಮದ್ಯಸಾರವನ್ನು ಮತ್ತು ಮೂರು ಗೋಣಿ ಚೀಲದಲ್ಲಿ 25 ರಟ್ಟಿನ ಪೆಟ್ಟಿಗೆಗಳಲ್ಲಿ ಖಾಲಿ ಸೀಸೆಗಳು, ಮೂರು ಪೆಟ್ಟಿಗೆಗಳಲ್ಲಿ ಕೊಡೇಸ್ ತ್ರಿಬಲ್ ಎಕ್ಸ್ ರಮ್ಮಿನ ಮುಚ್ಚಳಗಳು ಹಾಗೂ ವಾಹನ ಟಾಟಾ ಸುಮೋ ಸಂ: ಕೆ.ಎ-12-ಎಂ-3488 ರಲ್ಲಿ ಅಂದಾಜು 415 ಲೀ.

ಮದ್ಯಸಾರವನ್ನು ಹೊಂದಿರುವುದು ಕಂಡು ಬಂದಿರುತ್ತದೆ. ಸದರಿ ಮದ್ಯಸಾರವನ್ನು ಹೊಂದಿರುವುದು ಅಬಕಾರಿ ಕಾಯ್ದೆ ಪ್ರಕಾರ ಅಪರಾಧವಾಗಿರುವುದರಿಂದ ವಾಹನದ ಚಾಲಕನಾದ ಟಿ.ಪಿ.ಸಜೀವ, ತಂದೆ ತಂಗಚ್ಚನ್, ತಚ್ಚಂವಳ್ಳೀ ಹೌಸ್, ವೆಸ್ಟ್ ಎಳೆರಿ ಗ್ರಾಮ, ಬಮನಡಿ ಅಂಚೆ, ಹೊಸದುರ್ಗ, ಕಾನಂಗಾಡ್, ಕಾಸರಗೋಡು ಜಿಲ್ಲೆ, ಎರಡನೇ ದಾಸ್ ಹೊಸದುರ್ಗ, ಕಾಸರಗೋಡು ಜಿಲ್ಲೆ, ಕೇರಳ, ಮೂರನೇ ಆರೋಪಿ ಎಂ.ಜಿ. ನೀಲಾಂಬಿಕ, 'ಇ' ಬ್ಲಾಕ್, ಜೆ.ಪಿ. ನಗರ, ಮೈಸೂರು, ನಾಲ್ಕನೇ ಆರೋಪಿ ಮನೆ ಮಾಲೀಕರು ಇವರುಗಳ ಪೈಕಿ ಒಂದನೇ ಆರೋಪಿ ಸದರಿ ಅಪರಾಧ ಎಸಗಿರುವುದರಿಂದ ಒಂದನೇ ಆರೋಪಿಯನ್ನು ದಸ್ತಗಿರಿ ಮಾಡಲಾಗಿರುತ್ತದೆ. ವಾಹನದ ಚಾಲಕನನ್ನು ಸದರಿ ಮದ್ಯಸಾರವನ್ನು ಸಾಗಿಸಲು ಸರಕಾರದ ಪರವಾನಿಗೆ ಇದೆಯೇ ಎಂದು ವಿಚಾರಿಸಲಾಗಿ ಯಾವುದೂ ಇಲ್ಲವೆಂದು ತಿಳಿಸಿದ ಮೇರೆಗೆ ಅಕ್ರಮ ಸಾಗಾಣಿಕೆ ಎಂದು ಪರಿಗಣಿಸಿ ಕರ್ನಾಟಕ ರಾಜ್ಯ ಅಬಕಾರಿ ಕಾಯ್ದೆ 1965ರ ನಿಬಂಧನೆ 11,13,14 ರಂತೆ ಕಲಂ 32, 34, 38(ಎ) ರಂತೆ ಮೊಕದ್ದಮೆ ಸಂ: 29/2003-04, ದಿ: 25.2.04 ರಂತೆ ಮೊಕದ್ದಮೆ ದಾಖಲು ಮಾಡಿಕೊಂಡು ವಾಹನ ಟಾಟಾ ಸುಮೋ ಸಂಖ್ಯೆ:ಕೆಎ.-12-ಎಂ-3488 ಮತ್ತು ಅಕ್ರಮ ದಾಸ್ತಾನು ಹೊಂದಿದ್ದ ಮದ್ಯವನ್ನು ವಶಪಡಿಸಿಕೊಳ್ಳಲಾಗಿರುತ್ತದೆ. ದಾಖಲಿಸಲಾಗಿರುವ ಪ್ರಕರಣದ ತನಿಖೆ ಬಗ್ಗೆ ಪ್ರಕರಣವನ್ನು ಅಬಕಾರಿ ಉಪ ನಿರೀಕ್ಷಕರು, ಮಡಿಕೇರಿ ಉಪ ವಲಯ ಇವರಿಗೆ ಹಸ್ತಾರಿಸಿಕೊಟ್ಟಿರುತ್ತಾರೆ.

ಸದರಿ ವಶಪಡಿಸಿಕೊಂಡ ಮದ್ಯಸಾರದಿಂದ ರಾಸಾಯನಿಕ ಪರೀಕ್ಷೆಗೆ ಮಾದರಿ ತೆಗೆದು ದಿ: 23.3.04 ರಂದು ರಾಸಾಯನಿಕ ತಜ್ಞರು, ಮಂಗಳೂರು ಇವರಿಗೆ ಕಳುಹಿಸಲಾಗಿದ್ದು, ಅವರ ವರದಿ ದಿ: 16.7.04ರ ಪ್ರಕಾರ ಮದ್ಯಸಾರದ ಸಾಂದ್ರತೆಯು ಶೇಕಡಾ 94 ಹೊಂದಿದ್ದು, ಇದರಿಂದ ಮಾನವ ಸೇವನೆಗೆ ಯೋಗ್ಯವಿರುವುದಾಗಿ 415 ಲೀ. ಮದ್ಯಸಾರವನ್ನು ದಿ: 24.7.04 ರಂದು ಸರಕಾರಕ್ಕೆ ಮುಟ್ಟುಗೋಲು ಹಾಕಿಕೊಳ್ಳಲಾಗಿರುತ್ತದೆ. ಸದರಿ ವಾಹನದ ಮಾಲೀಕತ್ವವನ್ನು ಪತ್ತೆ ಹಚ್ಚಲು ದಿ:20.3.2004 ರಂದು ಪ್ರಾದೇಶಿಕ ಸಾರಿಗೆ ಅಧಿಕಾರಿಗಳು, ಕೊಡಗು ಜಿಲ್ಲೆ, ಮಡಿಕೇರಿ ರವರಿಗೆ ಪತ್ರ ಬರೆಯಲಾಗಿದ್ದು, ಅವರ ವರದಿಯಲ್ಲಿ ಸಿ.ಸಿ.ಯನ್ನು ಮೈಸೂರಿಗೆ ನೀಡಿರುವುದಾಗಿ ತಿಳಿಸಿರುತ್ತಾರೆ. ಆದ್ದರಿಂದ ದಿ:23.7.04 ರಂದು ಪ್ರಾದೇಶಿಕ ಸಾರಿಗೆ ಅಧಿಕಾರಿ ರವರಿಗೆ ಪತ್ರ ಬರೆಯಲಾಗಿದ್ದು, ಅವರಿಂದ ದಿ: 3.12.04 ರಂದು ಬಿ ಎಕ್ಸ್ಟ್ರ್ಯಾಕ್ಟ್ ಬಂದಿದ್ದು, ಅದರಲ್ಲಿ ನಮೂದಿಸಿದಂತೆ ಶ್ರೀಮತಿ ನೀಲಾಂಬಿಕ, ಗಂಡ ಎಸ್.ಸಿ. ಗುರುಸ್ವಾಮಿ, ನಂ:559, ಇ ಬ್ಲಾಕ್, ಮೂರನೇ ಕ್ರಾಸ್, ಜೆ.ಪಿ. ನಗರ, ಮೈಸೂರು ಇವರಿಗೆ ದಿ: 11.2.05 ರಂದು ಕರ್ನಾಟಕ ರಾಜ್ಯ ಅಬಕಾರಿ ಕಾಯ್ದೆ 1965ರ ಕಲಂ 43 ಬಿ ರ ಅಡಿಯಲ್ಲಿ ಕಾರಣ ಕೇಳಿಕೆ ನೋಟೀಸ್ ನೀಡಲಾಗಿತ್ತು. ಸದರಿ ನೋಟಿಸ್ ನೋಂದಣಿ ಅಂಚೆಯ ಮೂಲಕ ಕಳುಹಿಸಿದ್ದು, ಪತ್ರ ವಾಪಸ್ ಬಂದಿರುತ್ತದೆ. ನಂತರ ದಿ: 28.2.05 ರಂದು ಮರು ಪತ್ರ ನೋಂದಣಿ ಅಂಚೆಯ ಮೂಲಕ ಮೇಲೆ ಕಾಣಿಸಿದ ವಿಳಾಸದಾರರಿಗೆ ಕಾರಣ ಕೇಳಿ ನೋಟೀಸ್ ನೀಡಲಾಗಿದೆ.

ದಿನಾಂಕ: 10.3.05 ರಂದು ಶ್ರೀಮತಿ ನೀಲಾಂಬಿಕ ರವರು ಸದರಿ ಕಾರಣ ಕೇಳಿಕೆ ನೋಟೀಸಿಗೆ ಉತ್ತರವನ್ನು ನೀಡಿ ವಶಪಡಿಸಿಕೊಂಡ ವಾಹನವನ್ನು ಮಡಿಕೇರಿಯ ರೋಸ್ ಡಯಲ್ ಎಂಬ ಚಿಕ್ಕ ಕಛೇರಿಯಲ್ಲಿ ಸುರೇಶ್ ಇವರಿಂದ 2002ನೇ ಇಸವಿಯಲ್ಲಿ ಇವರ ಮುಖಾಂತರ ಲೋನಿನಲ್ಲಿ ಟಾಟಾ ಸುಮೋ ಸಂ: ಕೆ.ಎ.-12-ಎಂ-3488 ರನ್ನು ತೆಗೆದುಕೊಂಡಿದ್ದೆನು. ಕಾರಣಾಂತರದಿಂದ ಲೋನ್ ಕಟ್ಟಲು ಸಾಧ್ಯವಾಗದೇ ಇದ್ದುದರಿಂದ ಸುರೇಶ್ ಎಂಬುವರು 2003ನೇ ಇಸವಿ ಜುಲೈ ತಿಂಗಳಲ್ಲಿ ಟಾಟಾ ಸುಮೋವನ್ನು ನನ್ನಿಂದ ವಶಪಡಿಸಿಕೊಂಡಿರುವರು. ಆದುದರಿಂದ ನನ್ನ ಈಗಿನ ಆರ್ಥಿಕ ಸ್ಥಿತಿ ಸರಿಯಿಲ್ಲದ ಕಾರಣ ಲೋನ್ ಕಟ್ಟಲು ಸಾಧ್ಯವಿಲ್ಲದ್ದರಿಂದ ನನಗೂ ಈ ಮೊಕದ್ದಮೆಗೂ ಯಾವುದೇ ಸಂಬಂಧವಿರುವುದಿಲ್ಲವೆಂದು ಮೌಖಿಕವಾಗಿ ಈ ರೀತಿ ತಿಳಿಸಿರುತ್ತಾರೆ. ನನ್ನ ಆರ್ಥಿಕ ಸ್ಥಿತಿ ಸರಿಯಿಲ್ಲದ ಕಾರಣ ವಕೀಲರನ್ನು ನೇಮಿಸಿ ಮೊಕದ್ದಮೆಯನ್ನು ನಡೆಸಲು ನಾನು ಶಕ್ತಳಲ್ಲ ಆದುದರಿಂದ ವಾಹನವನ್ನು ಕಾನೂನು ರೀತಿ ವಿಲೇವಾರಿ ಮಾಡಲು ನನ್ನಿಂದ ಏನೂ ಅಭ್ಯಂತರವಿಲ್ಲವೆಂದು ಲಿಖಿತ ಮೂಲಕ ಪತ್ರ ಸಲ್ಲಿಸಿರುತ್ತಾರೆ.

ಆದುದರಿಂದ ಇನ್ನು ಹೆಚ್ಚು ಸಮಯ ಇಟ್ಟುಕೊಂಡಲ್ಲಿ ಗಾಳಿ ಮಳೆ ವಿಕೋಪಕ್ಕೆ ವಾಹನದ ಬಿಡಿ ಭಾಗಗಳು ತೀರಾ ಹಾಳಾಗುವ ಸಂಭವವಿರುವುದರಿಂದ ಹಾಗೂ ಅಧಿಕೃತ ಮಾಲೀಕರೇ ವಾಹನವನ್ನು ಕಾನೂನು ರೀತಿಯಲ್ಲಿ ವಿಲೇ ಮಾಡಲು ನನ್ನ ಅಭ್ಯಂತರವಿಲ್ಲವೆಂದು ಅರ್ಜಿ ಸಲ್ಲಿಸಿರುವುದರಿಂದ, ಹಾಗೂ ವಾಹನಗಳ ಶೀಘ್ರ ವಿಲೇವಾರಿ ದೃಷ್ಟಿಯಿಂದ, ಸರಕಾರದ ಆದಾಯದ ಹಿತದೃಷ್ಟಿಯಿಂದ, ಸರಕಾರಕ್ಕೆ ಮುಟ್ಟುಗೋಲು ಹಾಕಿಕೊಳ್ಳುವುದು ಸೂಕ್ತವೆಂದು ಪರಿಗಣಿಸಲಾಗಿದೆ.

ಹಾಗೂ ವಾಹನದ ಮಾಲೀಕರು ಸೂಕ್ತ ಸಾಕ್ಷ್ಯಾಧಾರಗಳೊಂದಿಗೆ ಪ್ರಾಧಿಕಾರಕ್ಕೆ ಹಾಜರಾಗಿ ಸಮಜಾಯಿಸಿಕೆಯನ್ನು ಸಲ್ಲಿಸಲು ವಿಫಲರಾಗಿರುವುದರಿಂದ ಹಾಗೂ ಅಬಕಾರಿ ಕಾನೂನಿನ ಅರಿವಿದ್ದೇ ಅಕ್ರಮ ಸಾಗಾಣಿಕೆಯಲ್ಲಿ ವಾಹನವನ್ನು ಬಳಸಿರುವುದು, ಮೇಲ್ನೋಟಕ್ಕೆ ಸಾಬೀತಾಗಿರುತ್ತದೆ. ಆದುದರಿಂದ ಸದರಿ ವಾಹನವನ್ನು ಸರಕಾರಕ್ಕೆ ಮುಟ್ಟುಗೋಲು ಹಾಕಿಕೊಳ್ಳುವುದು ಸೂಕ್ತವೆಂದು ಈ ಕೆಳಗಿನಂತೆ ಆದೇಶ.

**ಆದೇಶ ನಂ:ಇಎಕ್ಸ್ಇ:3:ಸಿಆರ್ಎಂ:185/2003-04, ದಿನಾಂಕ: 10ನೇ ಆಗಸ್ಟ್ 2005**

ಪ್ರಕರಣಕ್ಕೆ ಸಂಬಂಧಿಸಿ ಈ ಪ್ರಾಧಿಕಾರಕ್ಕೆ ಒಪ್ಪಿಸಲಾಗಿರುವ ದಾಖಲೆ ಪತ್ರಗಳನ್ನು ಹಾಗೂ ಪ್ರಸ್ತಾವನೆಯಲ್ಲಿ ವಿವರಿಸಲಾದ ಅಂಶಗಳನ್ನು ಪರಿಶೀಲಿಸಿ ಎನ್.ಎಂ. ಹುಸೇನ್, ಅಧಿಕೃತ ಅಧಿಕಾರಿ ಹಾಗೂ ಅಬಕಾರಿ ಅಧೀಕ್ಷಕರು ಇ.ಐ.ಬಿ, ಕೊಡಗು ಜಿಲ್ಲೆ, ಮಡಿಕೇರಿ ಆದ ನಾನು ಕರ್ನಾಟಕ ರಾಜ್ಯ ಅಬಕಾರಿ ಕಾಯ್ದೆ 1965ರ ಕಲಂ 43ಎ ಅಡಿಯಲ್ಲಿ ಸರ್ಕಾರದಿಂದ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ ಅಬಕಾರಿ ಉಪ ನಿರೀಕ್ಷಕರು, ಉಪ ವಿಭಾಗ, ಮಡಿಕೇರಿ ರವರ ಮೊಕದ್ದಮೆ ಸಂಖ್ಯೆ: 29/2003-04, ದಿ: 25.2.2004 ರಲ್ಲಿ ವಶಪಡಿಸಿಕೊಂಡ ಟಾಟಾ ಸುಮೋ ಸಂ:ಕೆ.ಎ.-12-ಎಂ-3488 ರನ್ನು ಕರ್ನಾಟಕ ರಾಜ್ಯ ಅಬಕಾರಿ ಕಾಯ್ದೆ 43ಸಿ ರನ್ವಯ ಸರಕಾರಕ್ಕೆ ಮುಟ್ಟುಗೋಲು ಹಾಕಿಕೊಂಡು ಆದೇಶ ನೀಡಿರುತ್ತೇನೆ.

ಈ ಆದೇಶವನ್ನು ಇಂದು ಅಂದರೆ ದಿ: 10.8.2005 ರಂದು ಶೀಘ್ರಲಿಪಿಗಾರರಿಗೆ ಉಕ್ತಲೇಖನ ಕೊಟ್ಟು ಬೆರಳಚ್ಚು ಮಾಡಿಸಿ ಕಂಪ್ಯೂಟರಿನಲ್ಲಿ ಮುದ್ರಿಸಿ, ಪ್ರತಿಯನ್ನು ತಿದ್ದಿ, ಮುಕ್ತ ನ್ಯಾಯಾಲಯದಲ್ಲಿ ಘೋಷಿಸಲಾಯಿತು.

ಈ ಆದೇಶ ಆದ 30 ದಿನಗಳ ನಂತರ ಮುಟ್ಟುಗೋಲು ಹಾಕಿಕೊಂಡ ವಾಹನವನ್ನು ಬಹಿರಂಗ ಹರಾಜು ಮೂಲಕ ಕರ್ನಾಟಕ ರಾಜ್ಯ ಅಬಕಾರಿ (ಮುಟ್ಟುಗೋಲು ಹಾಕಿಕೊಂಡ ವಸ್ತುಗಳ ವಿಲೇವಾರಿ) 1967ರ ನಿಯಮದಂತೆ ವಿಲೇವಾರಿ ಮಾಡಲು ಆದೇಶಿಸಿದೆ.

ಪಿ.ಆರ್. 1256 ಅಧಿಕೃತ ಅಧಿಕಾರಿಗಳು ಹಾಗೂ ಅಬಕಾರಿ ಅಧೀಕ್ಷಕರು, ಇ.ಐ.ಬಿ. ಕೊಡಗು ಜಿಲ್ಲೆ, ಮಡಿಕೇರಿ.

## ಕೈಮಗ್ಗ ಮತ್ತು ಜವಳಿ ಇಲಾಖೆ

## ಜವಳಿ ಅಭಿವೃದ್ಧಿ ಆಯುಕ್ತರ ಕಚೇರಿ, ನೃಪತುಂಗ ರಸ್ತೆ, ಬೆಂಗಳೂರು

**ಕಛೇರಿ ಆದೇಶ ಸಂಖ್ಯೆ:ಕೈಜಇ:ಅ:ಸಿ:ಸಿ4:2005-06, ದಿನಾಂಕ: 12ನೇ ಆಗಸ್ಟ್ 2005**

**ವಿಷಯ:** ಕೈಮಗ್ಗ ಮತ್ತು ಜವಳಿ ಇಲಾಖೆಯಲ್ಲಿ ಜವಳಿ ತನಿಖಾಧಿಕಾರಿಯ ಬ್ಯಾಕ್‌ಲಾಗ್ ಹುದ್ದೆಯ ನೇರ ನೇಮಕಾತಿ ಆದೇಶ.

**ಉಲ್ಲೇಖ:**
1. ಸರ್ಕಾರಿ ಅಧಿಸೂಚನೆ ಸಂಖ್ಯೆ:ಡಿ ಪಿ ಎ ಆರ್:13:ಎಸ್.ಬಿ.ಸಿ. 2001, ದಿನಾಂಕ: 21.11.2001.
2. ಸಮಾಜ ಕಲ್ಯಾಣ ಇಲಾಖೆಯ ಪತ್ರ ಸಂಖ್ಯೆ:ಬಿಅಂಡ್‌ಆರ್:ತಸ:ಸಿಆರ್:03-04, ದಿನಾಂಕ: 7.2.2004.

3. ಸರ್ಕಾರಿ ಪತ್ರ ಸಂಖ್ಯೆ:ವಾಕೈ:01:ಜಕೈಸೇ:2005, ದಿ:4.1.2005.
4. ಈ ಕಚೇರಿ ಅಧಿಸೂಚನೆ ಸಂಖ್ಯೆ:ಕೈಜಇ:ಆ:ಸಿ:ಸಿ4:04-05, ದಿನಾಂಕ: 21.2.2005.
5. ಸರ್ಕಾರದ ಅಧಿಸೂಚನೆ ಸಂಖ್ಯೆ:ಡಿಪಿಎಆರ್:13:ಎಸ್‌ಬಿಸಿ:2001, ದಿನಾಂಕ:1.6.2002.
6. ಕರ್ನಾಟಕ ರಾಜ್ಯ ಪತ್ರ ದಿನಾಂಕ 3.3.2005 ಹಾಗೂ 2.6.2005 ರಲ್ಲಿ ಪ್ರಕಟಣೆ.

ಉಲ್ಲೇಖ(1)ರ ಸರ್ಕಾರಿ ಅಧಿಸೂಚನೆಯಲ್ಲಿ ಕರ್ನಾಟಕ ನಾಗರೀಕ ಸೇವಾ ಪರಿಶಿಷ್ಟ ಜಾತಿ ಮತ್ತು ಪರಿಶಿಷ್ಟ ಪಂಗಡದವರಿಗೆ ಮೀಸಲಾದ ಹುದ್ದೆಗಳನ್ನು ತುಂಬದೇ ಇರುವಂತಹ ಖಾಲಿ ಹುದ್ದೆಗಳಿಗೆ (ವಿಶೇಷ ನೇಮಕಾತಿ) ನಿಯಮಾವಳಿ 2001 ಜಾರಿಗೊಳಿಸಲಾದ ಹಿನ್ನೆಲೆಯಲ್ಲಿ ಉಲ್ಲೇಖ (4)ರ ಈ ಕಚೇರಿಯ ಅಧಿಸೂಚನೆಯಲ್ಲಿ ಪರಿಶಿಷ್ಟ ಜಾತಿಯ ಒಂದು ಜವಳಿ ತನಿಖಾಧಿಕಾರಿಯ ನೇರ ನೇಮಕಾತಿ ಬ್ಯಾಕ್‌ಲಾಗ್ ಹುದ್ದೆಯನ್ನು ತುಂಬಲು ಅರ್ಜಿಗಳನ್ನು ಆಹ್ವಾನಿಸಲಾಗಿತ್ತು. ಅದರಂತೆ ಸ್ವೀಕೃತಿಯಾದ ಅರ್ಜಿಗಳನ್ನು ಉಲ್ಲೇಖ (1)ರ ಸರ್ಕಾರದ ಅಧಿಸೂಚನೆಯಲ್ಲಿನ ನಿಯಮಗಳಂತೆ ಪರಿಶೀಲಿಸಿ ಅರ್ಹತೆ ಆಧಾರದ ಮೇಲೆ ಈ ಕೆಳಕಾಣಿಸಿದ ಅಭ್ಯರ್ಥಿಯನ್ನು ವೇತನ ಶ್ರೇಣಿ ರೂ.4575-125-5700-150-7200-200-8400 ಮತ್ತು ಇತರೆ ಭತ್ಯೆಗಳು ಲಭ್ಯವಿರುವಂತೆ ಅವರ ಹೆಸರಿನ ಮುಂದೆ ಸೂಚಿಸಿರುವ ಕಚೇರಿಗೆ ಜವಳಿ ತನಿಖಾಧಿಕಾರಿ ಹುದ್ದೆಗೆ ತಾತ್ಕಾಲಿಕವಾಗಿ ನೇಮಕ ಮಾಡಿ ಆದೇಶಿಸಲಾಗಿದೆ ಹಾಗೂ ಸದರಿ ಅಭ್ಯರ್ಥಿಯು ಸಂಬಂಧಪಟ್ಟ ಜಿಲ್ಲಾ ಪಂಚಾಯತಿಯ ಅಧೀನಕ್ಕೆ ಒಳಪಟ್ಟಿರುತ್ತಾರೆ.

| ಅಭ್ಯರ್ಥಿಯ ಹೆಸರು ಮತ್ತು ವಿಳಾಸ | ಹುದ್ದೆ ಹಾಗೂ ನೇಮಕಾತಿ ಮಾಡಲಾದ ಕಚೇರಿ |
|---|---|
| 1. ಶ್ರೀ ಹೆಚ್. ಶಿವಶಂಕರ ಬಿನ್ ಹಲಗಯ್ಯ ಇ,<br>2ನೇ ಅಡ್ಡರಸ್ತೆ, ಕೆ.ಇ.ಬಿ. ಕಚೇರಿ, ಹತ್ತಿರ,<br>ಸಿದ್ದಯ್ಯನಗರ, ಬಿ.ಎಂ. ರಸ್ತೆ, ಹಾಸನ-573 201. | ಜವಳಿ ತನಿಖಾಧಿಕಾರಿ ಉಪನಿರ್ದೇಶಕರ ಕಛೇರಿ,<br>ಕೈಮಗ್ಗ ಮತ್ತು ಜವಳಿ ಇಲಾಖೆ,<br>ಜಿಲ್ಲಾ ಪಂಚಾಯತ್ ಬಾಗಲಕೋಟೆ ಜಿಲ್ಲೆ. |

ಈ ಅಭ್ಯರ್ಥಿಯು ಉಪನಿರ್ದೇಶಕರ ಕಚೇರಿ, ಕೈಮಗ್ಗ ಮತ್ತು ಜವಳಿ ಇಲಾಖೆ, ಜಿಲ್ಲಾ ಪಂಚಾಯತ್, ಬಾಗಲಕೋಟೆ ಜಿಲ್ಲೆ, ಇವರಲ್ಲಿ ಕರ್ತವ್ಯಕ್ಕೆ ಹಾಜರಾಗುವಂತೆ ಆದೇಶ ನೀಡಲಾಗಿದೆ. ಈ ಆದೇಶವು ಈ ಕೆಳಕಂಡ ಷರತ್ತು ಮತ್ತು ನಿಬಂಧನೆಗಳಿಗೆ ಒಳಪಟ್ಟಿರುತ್ತದೆ.

1. ಈ ಅಭ್ಯರ್ಥಿಯು ನೇಮಕಾತಿ ಆದೇಶ ಪಡೆದ 15 ದಿನದ ಅವಧಿಯಲ್ಲಿ ಕರ್ತವ್ಯಕ್ಕೆ ಹಾಜರಾಗತಕ್ಕದ್ದು, ತಪ್ಪಿದಲ್ಲಿ ಅಭ್ಯರ್ಥಿಯ ನೇಮಕಾತಿಯನ್ನು ರದ್ದುಪಡಿಸಲಾಗುವುದು.
2. ಈ ಅಭ್ಯರ್ಥಿಯು ನೇಮಕಾತಿ ಹೊಂದಿರುವ ಸ್ಥಳಕ್ಕೆ ಹೋಗಲು ಯಾವುದೇ ತರವಾದ ಪ್ರಯಾಣ ಭತ್ಯೆ ಅಥವಾ ಇನ್ನಾವುದೇ ಭತ್ಯೆಗಳಿಗೆ ಅರ್ಹನಾಗಿರುವುದಿಲ್ಲ.
3. ಈ ಅಭ್ಯರ್ಥಿಯು ಕರ್ತವ್ಯಕ್ಕೆ ಸೇರಿದ ದಿನಾಂಕದಿಂದ ಎರಡು ವರ್ಷಗಳ ಕಾಲ ಪದವಿಪೂರ್ವ ಅವಧಿಯಲ್ಲಿರುತ್ತಾರೆ.
4. ಕರ್ತವ್ಯಕ್ಕೆ ಸೇರುವ ಸಮಯದಲ್ಲಿ ಅಭ್ಯರ್ಥಿಯು ಈ ಕೆಳಗೆ ತಿಳಿಸಿರುವ ದಾಖಲೆಗಳನ್ನು ಸಂಬಂಧಪಟ್ಟ ಅಧಿಕಾರಿಗಳಿಗೆ ಒದಗಿಸತಕ್ಕದ್ದು.
   ಅ) ವಿದ್ಯಾರ್ಹತೆ (ಎಸ್.ಎಸ್.ಎಲ್.ಸಿ. ಮತ್ತು ಡಿಪ್ಲೋಮಾ ಬಗ್ಗೆ ಪ್ರಮಾಣ ಪತ್ರಗಳು)
   ಆ) ವಯಸ್ಸು ಹುಟ್ಟಿದ ದಿನಾಂಕದ ಬಗ್ಗೆ ಅಧಿಕೃತ ದಾಖಲೆ
   ಇ) ಜಿಲ್ಲಾ ಆರೋಗ್ಯಾಧಿಕಾರಿಗಳಿಂದ ದೇಹಸ್ಥಿತಿ ಬಗ್ಗೆ ಒಂದು ದೃಢೀಕರಣ ಪತ್ರ
   ಈ) ಮೂಲ ಜಾತಿ ಪತ್ರ
   ಉ) ಅಭ್ಯರ್ಥಿಯ ಸ್ಥಿರ ಮತ್ತು ಚರ ಆಸ್ತಿಗಳ ಬಗ್ಗೆ ದೃಢೀಕರಣ ಪತ್ರ
   ಊ) ವಿವಾಹಿತರಾಗಿದ್ದರೆ, ಒಂದಕ್ಕಿಂತ ಹೆಚ್ಚಾಗಿ ಜೀವಂತರಾಗಿರುವ ಪತ್ನಿಯನ್ನು ಪಡೆದಿಲ್ಲವೆಂದು ಪ್ರಮಾಣೀಕರಿಸುವ ದೃಢೀಕರಣ ಪತ್ರ
   ಋ) ಅಭ್ಯರ್ಥಿಯು ಭಾರತ ಸಂವಿಧಾನಕ್ಕೆ ನಿಷ್ಠೆಯಿಂದ ಸೇವೆ ಸಲ್ಲಿಸುವ ಬಗ್ಗೆ ಪ್ರಮಾಣ ಪತ್ರ.
   ೠ) ಅಭ್ಯರ್ಥಿಯು ಪದವಿಪೂರ್ವ ಅವಧಿಯಲ್ಲಿ ಜವಳಿ ತನಿಖಾಧಿಕಾರಿ ಹುದ್ದೆಗೆ ನಿಗದಿಪಡಿಸಿರುವ ಎಲ್ಲಾ ಇಲಾಖಾ ಪರೀಕ್ಷೆಗಳನ್ನು ತೇರ್ಗಡೆ ಮಾಡತಕ್ಕದ್ದು.
   ಎ) ಅಭ್ಯರ್ಥಿಯು ಒಂದು ವೇಳೆ ಈಗಾಗಲೇ ಉದ್ಯೋಗದಲ್ಲಿದ್ದರೆ ಸಂಬಂಧಪಟ್ಟ ಅವರ ಮೇಲಾಧಿಕಾರಿಗಳಿಂದ ಬಿಡುಗಡೆ ಪತ್ರವನ್ನು ಕರ್ತವ್ಯಕ್ಕೆ ಹಾಜರಾಗುವಾಗ ನೀಡುವುದು.

ಸಂಬಂಧಪಟ್ಟ ಅಧಿಕಾರಿಯವರು ಈ ಅಭ್ಯರ್ಥಿಯು ಕರ್ತವ್ಯಕ್ಕೆ ಹಾಜರಾದ ಕೂಡಲೇ ಮೇಲೆ ತಿಳಿಸಿದ ಎಲ್ಲಾ ದಾಖಲಾತಿಗಳನ್ನು ಪರಿಶೀಲಿಸಿ ಅಭ್ಯರ್ಥಿಯ ಹಾಜರಾತಿ ಮತ್ತು ದೃಢೀಕರಣ ಪತ್ರಗಳನ್ನು ಪರಿಶೀಲಿಸಿದ ಬಗ್ಗೆ ತಿಳಿಸಿದ ನಂತರ ಹೊಸ ಹುದ್ದೆಯ ದೃಢೀಕರಣ ಪತ್ರವನ್ನು ಈ ಕಚೇರಿಯಿಂದ ನೀಡಲಾಗುವುದು.

ಪಿ.ಆರ್. 1257 ಜವಳಿ ಅಭಿವೃದ್ಧಿ ಆಯುಕ್ತರು ಹಾಗೂ ನಿರ್ದೇಶಕರು, ಕೈಮಗ್ಗ ಮತ್ತು ಜವಳಿ

## ಸಹಕಾರ ಸಂಘಗಳ ಉಪ ನಿಬಂಧಕರ ಕಛೇರಿ, ಬೀದರ್ ಜಿಲ್ಲೆ, ಬೀದರ್

**ವಿಷಯ:** ಸಮಾಪನೆಗೊಂಡ ಹಾಲು ಉತ್ಪಾದಕರ ಸಹಕಾರ ಸಂಘ ನಿ, ಕುರುಬಖೇಳಗಿ ತಾ: ಭಾಲ್ಕಿ ಇದರ ನೊಂದಣಿ ಸಂಖ್ಯೆ ರದ್ದುಪಡಿಸುವ ಕುರಿತು.

**ಉಲ್ಲೇಖ:**
1. ಈ ಕಛೇರಿ ಆದೇಶ ಸಂಖ್ಯೆ:ಉನಿಬಿ/ವಿ1/ಸಮಾಪನೆ/99-2000 ದಿನಾಂಕ: 29.11.1999.
2. ಸಹಕಾರ ಸಂಘಗಳ ಸಹಾಯಕ ನಿಬಂಧಕರು, ಬೀದರ್ ಉಪ ವಿಭಾಗ, ಬೀದರ್ ಇವರ ಪತ್ರ ಸಂಖ್ಯೆ/ಸನಿಬಿ1/ವಿ1/ ಸಮಾಪನೆ/ ಸಿಆರ್-52/2004-2005/ದಿನಾಂಕ 26.7.2003 ಹಾಗೂ 11.8.05

**ಪ್ರಸ್ತಾವನೆ:**

ಹಾಲು ಉತ್ಪಾದಕರ ಸಹಕಾರ ಸಂಘ ನಿ, ಕುರುಬಖೇಳಗಿ ತಾಲ್ಲೂಕಾ ಭಾಲ್ಕಿ ಈ ಸಂಘವು ಸಂಖ್ಯೆ/ಎಆರ್-1/ಎಸ್-3/ಜೆಓಜಿ/15339/ 1988-89/ದಿನಾಂಕ:8.5.89ರಲ್ಲಿ ನೊಂದಣಿಯಾಗಿರುತ್ತದೆ. ಸಂಘದ ಕಾರ್ಯಚಟುವಟಿಕೆಗಳು ಪೂರ್ಣ ಸ್ಥಗಿತಗೊಂಡಿದ್ದರಿಂದ ಈ ಸಂಘವನ್ನು ಮುಂದುವರಿಸಿಕೊಂಡು ಹೋಗುವುದು ಸೂಕ್ತವಲ್ಲವೆಂದು ಭಾವಿಸಿ, ಉಲ್ಲೇಖ (1)ರ ಆದೇಶದಲ್ಲಿ ಸಮಾಪನೆಗೊಳಿಸಿ ಮಾರ್ಗ ವಿಸ್ತೀರ್ಣಾಧಿಕಾರಿ ಕೆ.ಎಂ.ಎಫ್. ಇವರನ್ನು ಸಮಾಪನಾಧಿಕಾರಿಯನ್ನಾಗಿ ನೇಮಕ ಮಾಡಲಾಗಿತ್ತು. ಸಮಾಪನಾಧಿಕಾರಿಗಳು ಸಂಘದ ನೊಂದಣಿ ಸಂಖ್ಯೆ ರದ್ದುಪಡಿಸಲು ಸಹಕಾರ ಸಂಘಗಳ ಸಹಾಯಕ ನಿಬಂಧಕರು, ಬೀದರ್ ಇವರ ಮೂಲಕ ಉಲ್ಲೇಖ (2)ರ ಮುಖೇನ ಪ್ರಸ್ತಾವನೆ ಸಲ್ಲಿಸಿರುತ್ತಾರೆ. ಸಹಕಾರ ಸಂಘಗಳ ಸಹಾಯಕ ನಿಬಂಧಕರು, ಬೀದರ್ ಇವರು ಸಂಘದಲ್ಲಿ ಯಾವುದೇ ಆಸ್ತಿ-ಜವಾಬ್ದಾರಿ ಇರುವುದಿಲ್ಲ ಮತ್ತು ಸಂಘದಿಂದ ಸರ್ಕಾರಕ್ಕೆ ಬರಬೇಕಾದ

ಯಾವುದೇ ಬಾಕಿ ಇಲ್ಲವೆಂದು ಪ್ರಮಾಣ ಪತ್ರ ನೀಡಿರುತ್ತಾರೆ. ಹಾಗೂ ಸಂಘದ ಹೆಸರಿನಲ್ಲಿ ಇರುವ ಶಿಲ್ಕು ಹಣವನ್ನು ಉಪ ನಿಬಂಧಕರ ಪಿ.ಡಿ. ಖಾತೆಗೆ ವರ್ಗಾಯಿಸಿ ಸಂಘದ ನೊಂದಣಿ ಸಂಖ್ಯೆ ರದ್ದುಪಡಿಸಲು ಶಿಫಾರಸ್ಸು ಮಾಡಿರುತ್ತಾರೆ. ಈ ಅಂಶಗಳನ್ನು ಪರಿಗಣಿಸಿ ಕೆಳಕಂಡ ಆದೇಶ ಹೊರಡಿಸಲಾಗಿದೆ.

**ಆದೇಶ**

**ಸಂಖ್ಯೆ/ಉನಿಬಿ/ವಿ2/ಸಮಾಪನೆ/ಸಿಆರ್- /2005-2006/2131, ದಿನಾಂಕ: 25ನೇ ಆಗಸ್ಟ್ 2005**

ಪ್ರಸ್ತಾವನೆಯಲ್ಲಿನ ಅಂಶಗಳನ್ನು ಪರಿಗಣಿಸಿ, ಕರ್ನಾಟಕ ಸಹಕಾರ ಸಂಘಗಳ ಕಾಯ್ದೆ 1959ರ ಕಲಂ 75 ರನ್ವಯ ಹಾಗೂ ಸರ್ಕಾರಿ ಅಧಿಸೂಚನೆ ಸಂಖ್ಯೆ ಸಿಎಂಡಬ್ಲ್ಯೂ/69/ಸಿಎಲ್ಎಂ/200/ದಿನಾಂಕ:21.11.2001 ರಲ್ಲಿ ದತ್ತವಾಗಿರುವ ಅಧಿಕಾರವನ್ನು ಚಲಾಯಿಸುತ್ತಾ **ಎಂ.ಡಿ. ಮಠಪತಿ** ಸಹಕಾರ ಸಂಘಗಳ ಉಪ ನಿಬಂಧಕರು, ಬೀದರ್ ಜಿಲ್ಲೆ ಬೀದರ್ ಆದ ನಾನು ಸಮಾಪನೆಗೊಂಡ ಹಾಲು ಉತ್ಪಾದಕರ ಸಹಕಾರ ಸಂಘ ನಿ, ಕುರುಬಖಳಗಿ ತಾ: ಭಾಲ್ಕಿ ಇದರ ನೊಂದಣಿ ಸಂಖ್ಯೆ/ಎಆರ್-1/ಎಸ್-3/ಜೆಓಜಿ/15339/1988-89/ದಿನಾಂಕ 8.5.1989 ನ್ನು ರದ್ದುಗೊಳಿಸಿ ಆದೇಶ ಹೊರಡಿಸಿರುತ್ತೇನೆ.

ಈ ರದ್ಧತಿಯ ಆದೇಶದ ದಿನಾಂಕದಿಂದ ಸದರಿ ಸಹಕಾರ ಸಂಘದ ಕಾರ್ಯಾಚಟುವಟಿಕೆಗಳು ನಿಂತುಹೋಗಿರುತ್ತವೆಂದು ಭಾವಿಸತಕ್ಕದ್ದು. ಈ ಸಂಘವು ಅಸ್ತಿತ್ವದಲ್ಲಿರುವುದಿಲ್ಲವೆಂದು ಪರಿಗಣಿಸತಕ್ಕದ್ದು. ಹಾಗೂ ಕರ್ನಾಟಕ ಸಹಕಾರ ಸಂಘಗಳ ನಿಯಮಗಳ 1960ರ ನಿಯಮ 33 (ಎನ್) ರನ್ವಯ ಈ ಸಂಘದ ದಾಖಲಾತಿಗಳನ್ನು ಸಹಕಾರ ಸಂಘಗಳ ಸಹಾಯಕ ನಿಬಂಧಕರು, ಬೀದರ್ ಇವರ ಕಛೇರಿಯಲ್ಲಿಡಲು ಆದೇಶಿಸಿದೆ.

ನನ್ನ ಸ್ವ ಸಹಿ ಮತ್ತು ಈ ಕಛೇರಿ ಮುದ್ರೆಯೊಂದಿಗೆ ದಿನಾಂಕ: 25.8.2005 ರಂದು ಈ ಆದೇಶವನ್ನು ಹೊರಡಿಸಲಾಗಿದೆ.

ಪಿ.ಆರ್. 1258 ಸಹಕಾರ ಸಂಘಗಳ ಉಪ ನಿಬಂಧಕರು, ಬೀದರ್.

## ಸಹಕಾರ ಸಂಘಗಳ ಉಪನಿಬಂಧಕರು, ದಾವಣಗೆರೆ ಜಿಲ್ಲೆ, ದಾವಣಗೆರೆ ಇವರ ಕಾರ್ಯಾಲಯ

**ವಿಷಯ:** ಸ್ಥಗಿತಗೊಂಡಿರುವ ಶಿವಶಕ್ತಿ ತೆಂಗಿನ ನಾರನ್ನು ಮತ್ತು ನಾರಿನ ಸರಕುಗಳನ್ನು ಉತ್ಪಾದಿಸುವ ಮತ್ತು ಮಾರಾಟ ಮಾಡುವ ಕೈಗಾರಿಕಾ ಸಹಕಾರ ಸಂಘ ನಿ, ಚಿನ್ನಮುಂಬಾಪುರ, ಹೊನ್ನಾಳಿ ತಾಲ್ಲೂಕು ಇದನ್ನು 1959ನೇ ಕರ್ನಾಟಕ ಸಹಕಾರ ಸಂಘಗಳ ಕಾಯ್ದೆ ಕಲಂ 72 ಮತ್ತು 73 ರನ್ವಯ ಸಮಾಪನೆಗೊಳಿಸುವ ಬಗ್ಗೆ.

**ಉಲ್ಲೇಖ:** 1. ಸಹಕಾರ ಸಂಘಗಳ ಸಹಾಯಕ ನಿಬಂಧಕರು, ದಾವಣಗೆರೆ ಇವರ ಪ್ರಸ್ತಾವನೆ ದಿನಾಂಕ: 14.7.2004.

2. ಈ ಕಛೇರಿಯ ಕಾರಣ ಕೇಳಿ ನೋಟೀಸ್ ಸಮ ಸಂಖ್ಯೆ ಪತ್ರ ದಿನಾಂಕ:11.8.2004.

**ಪ್ರಸ್ತಾವನೆ:**

ಸಹಕಾರ ಸಂಘಗಳ ಸಹಾಯಕ ನಿಬಂಧಕರು, ದಾವಣಗೆರೆ ಇವರು ಉಲ್ಲೇಖ (1)ರಲ್ಲಿ ಕಾಣಿಸಿದ ಪ್ರಸ್ತಾವನೆ ಪ್ರಕಾರ ಮೇಲ್ಕಂಡ ಸಂಘದ ಕಾರ್ಯಚಟುವಟಿಕೆಗಳು ಸ್ಥಗಿತಗೊಂಡಿರುತ್ತವೆ. ಸಂಘದ ಆಡಳಿತ ಸಮಿತಿಯವರು ಸಂಘದ ಅಭಿವೃದ್ಧಿ ಬಗ್ಗೆ ಗಮನಿಸುವಲ್ಲಿ ವಿಫಲವಾಗಿರುತ್ತದೆ ಮತ್ತು ಸಂಘವನ್ನು ಪುನಃಶ್ಚೇತನಗೊಳಿಸುವಲ್ಲಿ ಆಸಕ್ತಿ ಇರುವುದಿಲ್ಲ. ಈ ಬಗ್ಗೆ ಉಲ್ಲೇಖ (2)ರ ನೋಟೀಸು ನೀಡಿದ್ದು, ಇದಕ್ಕೆ ಯಾರಿಂದಲೂ ಪ್ರತಿಕ್ರಿಯೆ ಬಂದಿರುವುದಿಲ್ಲ. ಈ ಸಂಘದಿಂದ ಸದಸ್ಯರಿಗೆ ಯಾವ ರೀತಿಯ ಪ್ರಯೋಜನಾ ದೊರೆಯುತ್ತಿಲ್ಲ. ಸಂಘವನ್ನು ಇದೇ ರೀತಿ ಮುಂದುವರಿಯಲು ಬಿಟ್ಟಲ್ಲಿ ಸಂಘವು ಇನ್ನಷ್ಟು ಅಧೋಗತಿಗೆ ಹೋಗುವ ಸಂಭವವಿರುವುದರಿಂದ ಸಮಾಪನೆಗೊಳಿಸಲು ಸೂಕ್ತವೆಂದು ಕಂಡುಬಂದಿರುವುದರಿಂದ ಈ ಕೆಳಕಂಡ ಆದೇಶವನ್ನು ಹೊರಡಿಸಲಾಗಿದೆ.

**ಆದೇಶ**

**ನಂ:ಡಿಆರ್:ಡಿವಿಜಿ:ಎಲ್‌ಕ್ಯೂಡಿ:ಸಿಆರ್-32:2004-05, ದಿನಾಂಕ: 22ನೇ ಆಗಸ್ಟ್ 2005**

ಮೇಲ್ಕಂಡ ಪ್ರಸ್ತಾವನೆಯಲ್ಲಿ ವಿವರಿಸಿರುವಂತೆ ಮತ್ತು 1959ನೇ ಕರ್ನಾಟಕ ಸಹಕಾರ ಸಂಘಗಳ ಕಾಯ್ದೆ ಕಲಂ 72(2) ರನ್ವಯ ಸರ್ಕಾರದ ಅಧಿಸೂಚನೆ ಸಂಖ್ಯೆ:ಸಿಎಂಡಬ್ಲ್ಯೂ:69:ಸಿಎಲ್ಎಂ:2001, ದಿನಾಂಕ:21.11.2001ರ ಪ್ರಕಾರ ದತ್ತವಾದ ಅಧಿಕಾರದನ್ವಯ ದಾವಣಗೆರೆ ಜಿಲ್ಲಾ ಸಹಕಾರ ಸಂಘಗಳ ಉಪನಿಬಂಧಕರು ಕೆ.ಎಂ. ಆಶಾ ಕೆ.ಸಿ.ಎಸ್. ಆದ ನಾನು ನನಗೆ ದತ್ತವಾದ ಅಧಿಕಾರವನ್ನು ಚಲಾಯಿಸುತ್ತಾ, ಶಿವಶಕ್ತಿ ತೆಂಗಿನ ನಾರನ್ನು ಮತ್ತು ನಾರಿನ ಸರಕುಗಳನ್ನು ಉತ್ಪಾದಿಸುವ ಮತ್ತು ಮಾರಾಟ ಮಾಡುವ ಕೈಗಾರಿಕಾ ಸಹಕಾರ ಸಂಘ ನಿ, ಚಿನ್ನಮುಂಬಾಪುರ, ಹೊನ್ನಾಳಿ ತಾಲ್ಲೂಕು ಇದನ್ನು ಸಮಾಪನೆಗೊಳಿಸಿ 1959ನೇ ಕರ್ನಾಟಕ ಸಹಕಾರ ಸಂಘಗಳ ಕಾಯ್ದೆ ಕಲಂ 73(1) ರನ್ವಯ ಸಹಕಾರ ಅಭಿವೃದ್ಧಿ ಅಧಿಕಾರಿ ಹೊನ್ನಾಳಿ ಇವರನ್ನು ಸಂಘದ ಸಮಾಪನಾಧಿಕಾರಿಯನ್ನಾಗಿ ಅಧಿಕ ಪ್ರಭಾರದಲ್ಲಿ ನೇಮಿಸಿರುತ್ತೇನೆ. ಸಮಾಪನಾಧಿಕಾರಿಯು ಸಂಘದ ವಿಶಿಷ್ಟ ಪ್ರಭಾರವನ್ನು ಮತ್ತು ಸಂಘದ ಆಸ್ತಿಗಳನ್ನು ಸಂಘದ ಕಾರ್ಯದರ್ಶಿ ಅಥವಾ ಸಂಘದ ಪ್ರಭಾರ ಹೊಂದಿದ ಯಾವುದೇ ವ್ಯಕ್ತಿಯಿಂದ 1959ನೇ ಕರ್ನಾಟಕ ಸಹಕಾರ ಸಂಘಗಳ ಕಾಯ್ದೆ ಕಲಂ 73(1) ಮತ್ತು 74ರ ನಿಯಮದ ಪ್ರಕಾರ ಪಡೆದುಕೊಳ್ಳತಕ್ಕದ್ದು.

ನನ್ನ ಸ್ವಹಸ್ತ ಸಹಿ ಮತ್ತು ಕಛೇರಿ ಮುದ್ರೆಯೊಂದಿಗೆ ಈ ದಿನ ದಿನಾಂಕ: 22.8.2005 ರಂದು ಈ ಆದೇಶವನ್ನು ಹೊರಡಿಸಿರುತ್ತೇನೆ.

ಪಿ.ಆರ್. 1260 ಸಹಕಾರ ಸಂಘಗಳ ಉಪನಿಬಂಧಕರು, ದಾವಣಗೆರೆ ಜಿಲ್ಲೆ, ದಾವಣಗೆರೆ.

## ಪ್ರಾದೇಶಿಕ ಸಾರಿಗೆ ಅಧಿಕಾರಿಗಳು ಹಾಗೂ ನೊಂದಣಿ ಪ್ರಾಧಿಕಾರ, ಚಿಕ್ಕಮಗಳೂರು ಇವರ ನಡವಳಿ

**ಉಪಸ್ಥಿತರು:** ಶ್ರೀ ಆರ್. ರಾಜಶೇಖರ್,
ಪ್ರಾದೇಶಿಕ ಸಾರಿಗೆ ಅಧಿಕಾರಿಗಳು, ಹಾಗೂ ನೊಂದಣಿ ಪ್ರಾಧಿಕಾರ, ಚಿಕ್ಕಮಗಳೂರು.

**ವಿಷಯ:** ಕೆಎ-16:909 (ಸ್ಟೇ:ಕ್ಯಾ) ಇದರ ನೊಂದಣಿ ರದ್ದುಪಡಿಸುವ ಬಗ್ಗೆ.

**ಉಲ್ಲೇಖ:** 1. ಮಾಲೀಕರು ಶ್ರೀ ಹೆಚ್.ಆರ್. ಷಣ್ಮುಖ, ಚಿಕ್ಕಮಗಳೂರು ಇವರ ಅರ್ಜಿ ದಿನಾಂಕ:21.7.05.

2. ಅಧ್ಯರ್ಪಣ ಸಂ: 19.2.2003 ದಿ:4.7.02.

3. ಮೋಟಾರು ವಾಹನ ನಿರೀಕ್ಷಕರ ವರದಿ ದಿ: 22.7.03.

ಈ ಕಛೇರಿಯ ದಾಖಲೆಗಳಂತೆ ವಾಹನ ಸಂ: ಕೆಎ-16:909 (ಸ್ಟೇ:ಕ್ಯಾ) ಇದರ ನೊಂದಾಯಿತ ಮಾಲೀಕರಾದ ಶ್ರೀ ಹೆಚ್.ಆರ್. ಷಣ್ಮುಖ, ಚಿಕ್ಕಮಗಳೂರು ರವರು ಸದರಿ ವಾಹನದ ತೆರಿಗೆಯನ್ನು 31.7.02 ವರೆಗೆ ಪಾವತಿಸಿ ಮುಂದಿನ ತೆರಿಗೆಯಿಂದ ವಿನಾಯಿತಿ ಪಡೆಯಲು ಸದರಿ ವಾಹನದ ಅನುಪಯೋಗದ ಮಾಹಿತಿ ನೀಡಿ ಕಛೇರಿಗೆ ವಾಹನದ ಎಲ್ಲಾ ದಾಖಲೆಗಳನ್ನು ಅಧ್ಯರ್ಪಣ ಸಂ:19.2.03 ರಲ್ಲಿ ದಿ: 4.7.2002 ರಿಂದ ಅಧ್ಯರ್ಪಣ ಮಾಡಿದ್ದು, ಇಂದಿಗೂ ಅಧ್ಯರ್ಪಣ ಮುಂದುವರೆದಿದೆ.

ಕಛೇರಿಗೆ ದಿ: 21.7.2005 ರಂದು ಅರ್ಜಿ ಸಲ್ಲಿಸಿ ಈ ವಾಹನವು 1990 ರ ಮಾಡೆಲ್ ಆಗಿದ್ದು ರಸ್ತೆಯಲ್ಲಿ ಓಡಿಸಲು ಅನರ್ಹವಿರುವುದಾಗಿ ಮಾಹಿತಿ ನೀಡಿ ನೊಂದಣಿ ರದ್ದುಪಡಿಸಲು ಕೋರಿರುತ್ತಾರೆ. ಪೂರಕವಾಗಿ ಈ ಕಛೇರಿಯಿಂದ ಮೋಟಾರು ವಾಹನ ನಿರೀಕ್ಷಕರವರು ಈ ವಾಹನದ ಸ್ಥಿತಿಗತಿ ಪರಿಶೀಲಿಸಿ ಕಛೇರಿಗೆ ದಿ:22.7.2003 ರಂದು ಸಲ್ಲಿಸಿದ ವರದಿಯಲ್ಲಿ ಈ ವಾಹನದ ನೊಂದಣಿ ರದ್ದುಪಡಿಸಲು ಶಿಫಾರಸ್ಸು ಮಾಡಿರುತ್ತಾರೆ. ಅದರಂತೆ ನೊಂದಣಿ ರದ್ದುಪಡಿಸಲು ಈ ಕೆಳಗಿನಂತೆ ಆದೇಶ ಮಾಡಿದೆ.

**ಆದೇಶ**

**ಸಂ:ಪ್ರಾಸಾಅ:ಚಿಮ:ಎಫ್‌ಟಿ:ಸಾರಿಗೆ:04-05:06 ದಿನಾಂಕ: 26ನೇ ಜುಲೈ 2005**

ಕೇಂದ್ರ ಮೋಟಾರು ವಾಹನ ಕಾಯಿದೆ, 1988ರ ಕಲಂ 55ರಲ್ಲಿ ದತ್ತವಾದ ಅಧಿಕಾರದ ಮೇರೆಗೆ ಶ್ರೀ ಆರ್ ರಾಜಶೇಖರ್, ಪ್ರಾದೇಶಿಕ ಸಾರಿಗೆ ಅಧಿಕಾರಿ ಹಾಗೂ ನೊಂದಣಿ ಪ್ರಾಧಿಕಾರ, ಚಿಕ್ಕಮಗಳೂರು ಆದ ನಾನು ವಾಹನ ಸಂ: ಕೆಎ-16:909 (ಸ್ಟೇ:ಕ್ಯಾ) ವಾಹನದ ನೊಂದಣಿ ಹಾಗೂ ನೊಂದಣಿ ಪತ್ರವನ್ನು ಸದರಿ ವಾಹನದ ಮೇಲೆ ಮುಂದೆ ಲೆಕ್ಕ ಪರಿಶೋಧನೆಯಿಂದ ಬರಬೇಕಾದ ಬಾಕಿ ಏನಾದರೂ ಕಂಡುಬಂದಲ್ಲಿ ವಾಹನದ ಮಾಲೀಕರು ಪಾವತಿಸಲು ಬದ್ಧರಿರುತ್ತಾರೆಂಬ ಷರತ್ತಿನ ಮೇಲೆ ನೊಂದಣಿಯಮನ್ನು ರದ್ದುಪಡಿಸಿರುತ್ತೇನೆ.

**ವಾಹನದ ವಿವರಗಳು:**

| | | | |
|---|---|---|---|
| 1. | ವಾಹನ ಸಂ | : | ಕೆಎ-16:909 |
| 2. | ವರ್ಗ | : | ಸ್ಟೇ:ಕ್ಯಾ |
| 3. | ಮಾಡೆಲ್ | : | 1990 |
| 4. | ತಯಾರಿಕೆ | : | 1990 |
| 5. | ಚಾಸಿಸ್ ಸಂ | : | 344050 347190 |
| 6. | ಯಂತ್ರಸಂ | : | 692 ಡಿ 2335 8258 |
| 7. | ತೆರಿಗೆ ಪಾವತಿ | : | 31.7.2002 ಎಸ್ ಆರ್ ದಿ: 4.7.02 ದಿಂದ ಜಾರಿಗೆ. |
| 8. | ಹೆಚ್ ಪಿ ಎ | : | ಇರುವುದಿಲ್ಲ. |
| 9. | ನೊಂದಣಿ ದಿ | : | 1.8.90 |
| 10. | ಎಸ್ ಆರ್ ಸಂ | : | ಇಲ್ಲ |
| 11. | ಮಾಲೀಕರು | : | ಶ್ರೀ ಹೆಚ್.ಆರ್. ಷಣ್ಮುಖ ಬಿನ್ ಲೇ. ಹೆಚ್.ಬಿ. ರಾಮೇಗೌಡ, ಅರವಿಂದ ನಗರ, ಚಿಕ್ಕಮಗಳೂರು. |

**ಆರ್. ರಾಜಶೇಖರ್**

ಪಿ.ಆರ್. 1261 ಪ್ರಾದೇಶಿಕ ಸಾರಿಗೆ ಅಧಿಕಾರಿ ಹಾಗೂ ನೊಂದಣಿ ಪ್ರಾಧಿಕಾರ, ಚಿಕ್ಕಮಗಳೂರು.

**ಪ್ರಾದೇಶಿಕ ಸಾರಿಗೆ ಅಧಿಕಾರಿಗಳು ಹಾಗೂ ನೊಂದಣಿ ಪ್ರಾಧಿಕಾರ, ಚಿಕ್ಕಮಗಳೂರು ಇವರ ನಡವಳಿ**

**ಉಪಸ್ಥಿತರು:** ಶ್ರೀ ಆರ್. ರಾಜಶೇಖರ್,
ಪ್ರಾದೇಶಿಕ ಸಾರಿಗೆ ಅಧಿಕಾರಿಗಳು, ಹಾಗೂ ನೊಂದಣಿ ಪ್ರಾಧಿಕಾರ, ಚಿಕ್ಕಮಗಳೂರು.

**ವಿಷಯ:** ಕೆಎ-18:3618 (ಸ್ಟೇ:ಕ್ಯಾ) ಇದರ ನೊಂದಣಿ ರದ್ದುಪಡಿಸುವ ಬಗ್ಗೆ.

**ಉಲ್ಲೇಖ:** 1. ಮಾಲೀಕರು ಶ್ರೀಮತಿ ಅನುಪ, ಉಪ್ಪಳ್ಳಿ, ಚಿಕ್ಕಮಗಳೂರು ಇವರ ಅರ್ಜಿ ದಿನಾಂಕ:17.7.03.
2. ಅಧ್ಯರ್ಪಣ ಸಂ: 31:02-03 ದಿ:30.8.02.
3. ಮೋಟಾರು ವಾಹನ ನಿರೀಕ್ಷಕರ ವರದಿ ದಿ: 5.10.02.

ಈ ಕಛೇರಿಯ ದಾಖಲೆಗಳಂತೆ ವಾಹನ ಸಂ: ಕೆಎ-18:3618 (ಸ್ಟೇ:ಕ್ಯಾ) ಇದರ ನೊಂದಾಯಿತ ಮಾಲೀಕರಾದ ಶ್ರೀಮತಿ ಅನುಪ ಉಪ್ಪಳ್ಳಿ, ಚಿಕ್ಕಮಗಳೂರು ರವರು ಸದರಿ ವಾಹನದ ತೆರಿಗೆಯನ್ನು 31.8.02 ವರೆಗೆ ಪಾವತಿಸಿ ಮುಂದಿನ ತೆರಿಗೆಯಿಂದ ವಿನಾಯಿತಿ ಪಡೆಯಲು ಸದರಿ ವಾಹನದ ಅನುಪಯೋಗದ ಮಾಹಿತಿ ನೀಡಿ ಕಛೇರಿಗೆ ವಾಹನದ ಎಲ್ಲಾ ದಾಖಲೆಗಳನ್ನು ಅಧ್ಯರ್ಪಣ ಸಂ:31:02-03 ರಲ್ಲಿ ದಿ: 30.8.02 ರಿಂದ ಅಧ್ಯರ್ಪಣ ಮಾಡಿದ್ದು, ಇಂದಿಗೂ ಅಧ್ಯರ್ಪಣ ಮುಂದುವರೆದಿದೆ.

ಮಾಲೀಕರು ಕಛೇರಿಗೆ ದಿ: 17.7.03 ರಂದು ಅರ್ಜಿ ಸಲ್ಲಿಸಿ ಈ ವಾಹನವು 1986 ರ ಮಾಡೆಲ್ ಆಗಿದ್ದು ರಸ್ತೆಯಲ್ಲಿ ಓಡಿಸಲು ಅನರ್ಹವಿರುವುದಾಗಿ ಮಾಹಿತಿ ನೀಡಿ ನೊಂದಣಿ ರದ್ದುಪಡಿಸಲು ಕೋರಿರುತ್ತಾರೆ. ಪೂರಕವಾಗಿ ಈ ಕಛೇರಿಯಿಂದ ಮೋಟಾರು ವಾಹನ ನಿರೀಕ್ಷಕರವರು ಈ ವಾಹನದ ಸ್ಥಿತಿಗತಿ ಪರಿಶೀಲಿಸಿ ಕಛೇರಿಗೆ ದಿ:17.7.2003 ರಂದು ಸಲ್ಲಿಸಿದ ವರದಿಯಲ್ಲಿ ಈ ವಾಹನದ ನೊಂದಣಿ ರದ್ದುಪಡಿಸಲು ಶಿಫಾರಸ್ಸು ಮಾಡಿರುತ್ತಾರೆ. ಅದರಂತೆ ನೊಂದಣಿ ರದ್ದುಪಡಿಸಲು ಈ ಕೆಳಗಿನಂತೆ ಆದೇಶ ಮಾಡಿದೆ.

**ಆದೇಶ**

**ಸಂ:ಪ್ರಾಸಾಅ:ಚಿಮ:ಎಫ್‌ಟಿ:ಸಾರಿಗೆ:04-05, ದಿನಾಂಕ: 23ನೇ ಜುಲೈ 2005**

ಕೇಂದ್ರ ಮೋಟಾರು ವಾಹನ ಕಾಯಿದೆ, 1988ರ ಕಲಂ 55ರಲ್ಲಿ ದತ್ತವಾದ ಅಧಿಕಾರದ ಮೇರೆಗೆ ಶ್ರೀ ಆರ್ ರಾಜಶೇಖರ್, ಪ್ರಾದೇಶಿಕ ಸಾರಿಗೆ ಅಧಿಕಾರಿ ಹಾಗೂ ನೊಂದಣಿ ಪ್ರಾಧಿಕಾರ, ಚಿಕ್ಕಮಗಳೂರು ಆದ ನಾನು ವಾಹನ ಸಂ: ಕೆಎ-18:3618 (ಸ್ಟೇ:ಕ್ಯಾ) ವಾಹನದ ನೊಂದಣಿ ಹಾಗೂ ನೊಂದಣಿ ಪತ್ರವನ್ನು ಸದರಿ ವಾಹನದ ಮೇಲೆ ಮುಂದೆ ಲೆಕ್ಕ ಪರಿಶೋಧನೆಯಿಂದ ಬರಬೇಕಾದ ಬಾಕಿ ಏನಾದರೂ ಕಂಡುಬಂದಲ್ಲಿ ವಾಹನದ ಮಾಲೀಕರು ಪಾವತಿಸಲು ಬದ್ಧರಿರುತ್ತಾರೆಂಬ ಷರತ್ತಿನ ಮೇಲೆ ನೊಂದಣಿಯನ್ನು ರದ್ದುಪಡಿಸಿರುತ್ತೇನೆ.

**ವಾಹನದ ವಿವರಗಳು:**

| | | | |
|---|---|---|---|
| 1. | ವಾಹನ ಸಂ | : | ಕೆಎ-18:3618 |
| 2. | ವರ್ಗ | : | ಸ್ಟೇ:ಕ್ಯಾ |
| 3. | ಮಾಡೆಲ್ | : | 1986 |
| 4. | ತಯಾರಿಕೆ | : | 1986 |
| 5. | ಚಾಸಿಸ್ ಸಂ | : | 344068 220905 |

6. ಯಂತ್ರಸಂ : 692 ಡಿ 032 28660
7. ತೆರಿಗೆ ಪಾವತಿ : 31.8.02
8. ಹೆಚ್ ಪಿ ಎ : ಇಲ್ಲ.
9. ನೊಂದಣಿ ದಿ : 18.6.86
10. ಎಸ್ ಆರ್ ಸಂ : 31:02-03
11. ಮಾಲೀಕರು : ಶ್ರೀಮತಿ ಅನುಪ ಕೋಂ ಹೆಚ್.ಆರ್. ಷಣ್ಮುಖ, ಉಪ್ಪಳ್ಳಿ, ಚಿಕ್ಕಮಗಳೂರು.

**ಆರ್. ರಾಜಶೇಖರ್**

ಪಿ.ಆರ್. 1262 ಪ್ರಾದೇಶಿಕ ಸಾರಿಗೆ ಅಧಿಕಾರಿ ಹಾಗೂ ನೊಂದಣಿ ಪ್ರಾಧಿಕಾರ, ಚಿಕ್ಕಮಗಳೂರು.

## ಸಹಕಾರ ಸಂಘಗಳ ಉಪ ನಿಬಂಧಕರ ಕಛೇರಿ, ಬೀದರ್ ಜಿಲ್ಲೆ, ಬೀದರ್

**ವಿಷಯ:** ಸಮಾಪನೆಗೊಂಡ ಹಾಲು ಉತ್ಪಾದಕರ ಸಹಕಾರ ಸಂಘ ನಿ, ಹುಲಸೂರು ತಾ: ಬಸವಕಲ್ಯಾಣ ಇದರ ನೊಂದಣಿ ಸಂಖ್ಯೆ ರದ್ದುಪಡಿಸುವ ಕುರಿತು.

**ಉಲ್ಲೇಖ:** 1. ಈ ಕಛೇರಿ ಆದೇಶ ಸಂಖ್ಯೆ:ಉನಿಬಿ/ವಿ1/ಸಮಾಪನೆ/98-1999 ದಿನಾಂಕ: 17.11.1998.
2. ಸಹಕಾರ ಸಂಘಗಳ ಸಹಾಯಕ ನಿಬಂಧಕರು, ಬೀದರ್ ಉಪ ವಿಭಾಗ, ಬೀದರ್ ಇವರ ಪತ್ರ ಸಂಖ್ಯೆ/ಸನಿಬಿ1/ವಿ6/ಸಮಾಪನೆ/ 2005-2006/ದಿನಾಂಕ 16.8.2003.

**ಪ್ರಸ್ತಾವನೆ:**

ಹಾಲು ಉತ್ಪಾದಕರ ಸಹಕಾರ ಸಂಘ ನಿ, ಹುಲಸೂರು ತಾಲ್ಲೂಕಾ ಬಸವಕಲ್ಯಾಣ ಈ ಸಂಘವು ಸಂಖ್ಯೆ/ಎಆರ್-1/ಪಿಎಸ್ಆರ್/ಬಿಡಿಆರ್/ಎಂಪಿಸಿಎಸ್/7416/79-80 ದಿನಾಂಕ:8.4.79ರಲ್ಲಿ ನೊಂದಣಿಯಾಗಿರುತ್ತದೆ. ಸಂಘದ ಕಾರ್ಯಚಟುವಟಿಕೆಗಳು ಪೂರ್ಣ ಸ್ಥಗಿತಗೊಂಡಿದ್ದರಿಂದ ಈ ಸಂಘವನ್ನು ಮುಂದುವರಿಸಿಕೊಂಡು ಹೋಗುವುದು ಸೂಕ್ತವಲ್ಲವೆಂದು ಭಾವಿಸಿ, ಉಲ್ಲೇಖ (1)ರ ಆದೇಶದಲ್ಲಿ ಸಮಾಪನೆಗೊಳಿಸಿ ಮಾರ್ಗ ವಿಸ್ತೀರ್ಣಾಧಿಕಾರಿ ಕೆ.ಎಂ.ಎಫ್. ಇವರನ್ನು ಸಮಾಪನಾಧಿಕಾರಿಯನ್ನಾಗಿ ನೇಮಕ ಮಾಡಲಾಗಿತ್ತು. ಸಮಾಪನಾಧಿಕಾರಿಗಳು ಸಂಘದ ನೊಂದಣಿ ಸಂಖ್ಯೆ ರದ್ದುಪಡಿಸಲು ಸಹಕಾರ ಸಂಘಗಳ ಸಹಾಯಕ ನಿಬಂಧಕರು, ಬೀದರ್ ಇವರ ಮೂಲಕ ಉಲ್ಲೇಖ (2)ರ ಮುಖೇನ ಪ್ರಸ್ತಾವನೆ ಸಲ್ಲಿಸಿರುತ್ತಾರೆ. ಸಹಕಾರ ಸಂಘಗಳ ಸಹಾಯಕ ನಿಬಂಧಕರು, ಬೀದರ್ ಇವರು ಸಂಘದಲ್ಲಿ ಯಾವುದೇ ಆಸ್ತಿ-ಜವಾಬ್ದಾರಿ ಇರುವುದಿಲ್ಲ ಮತ್ತು ಸಂಘದಿಂದ ಸರ್ಕಾರಕ್ಕೆ ಬರಬೇಕಾದ ಯಾವುದೇ ಬಾಕಿ ಇಲ್ಲವೆಂದು ಪ್ರಮಾಣ ಪತ್ರ ನೀಡಿರುತ್ತಾರೆ. ಹಾಗೂ ಸಂಘದ ಹೆಸರಿನಲ್ಲಿ ಇರುವ ಶಿಲ್ಕು ಹಣವನ್ನು ಉಪ ನಿಬಂಧಕರ ಪಿ.ಡಿ. ಖಾತೆಗೆ ವರ್ಗಾಯಿಸಿ ಸಂಘದ ನೊಂದಣಿ ಸಂಖ್ಯೆ ರದ್ದುಪಡಿಸಲು ಶಿಫಾರಸ್ಸು ಮಾಡಿರುತ್ತಾರೆ. ಈ ಅಂಶಗಳನ್ನು ಪರಿಗಣಿಸಿ ಕೆಳಕಂಡ ಆದೇಶ ಹೊರಡಿಸಲಾಗಿದೆ.

### ಆದೇಶ

### ಸಂಖ್ಯೆ/ಉನಿಬಿ/ವಿ2/ಸಮಾಪನೆ/ಸಿಆರ್- /2005-2006/2155, ದಿನಾಂಕ: 26ನೇ ಆಗಸ್ಟ್ 2005

ಪ್ರಸ್ತಾವನೆಯಲ್ಲಿನ ಅಂಶಗಳನ್ನು ಪರಿಗಣಿಸಿ, ಕರ್ನಾಟಕ ಸಹಕಾರ ಸಂಘಗಳ ಕಾಯ್ದೆ 1959ರ ಕಲಂ 75 ರನ್ವಯ ಹಾಗೂ ಸರ್ಕಾರಿ ಅಧಿಸೂಚನೆ ಸಂಖ್ಯೆ ಸಿಎಂಡಬ್ಲ್ಯೂ/69/ಸಿಎಲ್ಎಂ/200/ದಿನಾಂಕ:21.11.2001 ರಲ್ಲಿ ದತ್ತವಾಗಿರುವ ಅಧಿಕಾರವನ್ನು ಚಲಾಯಿಸುತ್ತಾ **ಎಂ.ಡಿ. ಮಠಪತಿ** ಸಹಕಾರ ಸಂಘಗಳ ಉಪ ನಿಬಂಧಕರು, ಬೀದರ್ ಜಿಲ್ಲೆ ಬೀದರ್ ಆದ ನಾನು ಸಮಾಪನೆಗೊಂಡ ಹಾಲು ಉತ್ಪಾದಕರ ಸಹಕಾರ ಸಂಘ ನಿ, ಹುಲಸೂರು ತಾ।। ಬಸವಕಲ್ಯಾಣ ಇದರ ನೊಂದಣಿ ಸಂಖ್ಯೆ/ಎಆರ್-1/ಪಿಎಸ್ಆರ್/ಬಿಡಿಆರ್/ಎಂಪಿಸಿಎಸ್/7416/79-80 ದಿನಾಂಕ:8.4.79 ನ್ನು ರದ್ದುಗೊಳಿಸಿ ಆದೇಶ ಹೊರಡಿಸಿರುತ್ತೇನೆ.

ಈ ರದ್ದತಿಯ ಆದೇಶದ ದಿನಾಂಕದಿಂದ ಸದರಿ ಸಹಕಾರ ಸಂಘದ ಕಾರ್ಯಾಚಟುವಟಿಕೆಗಳು ನಿಂತುಹೋಗಿರುತ್ತವೆಂದು ಭಾವಿಸತಕ್ಕದ್ದು. ಈ ಸಂಘವು ಅಸ್ತಿತ್ವದಲ್ಲಿರುವುದಿಲ್ಲವೆಂದು ಪರಿಗಣಿಸತಕ್ಕದ್ದು. ಹಾಗೂ ಕರ್ನಾಟಕ ಸಹಕಾರ ಸಂಘಗಳ ನಿಯಮಗಳ 1960ರ ನಿಯಮ 33 (ಎನ್) ರನ್ವಯ ಈ ಸಂಘದ ದಾಖಲಾತಿಗಳನ್ನು ಸಹಕಾರ ಸಂಘಗಳ ಸಹಾಯಕ ನಿಬಂಧಕರು, ಬೀದರ್ ಇವರ ಕಛೇರಿಯಲ್ಲಿಡಲು ಆದೇಶಿಸಿದೆ.

ನನ್ನ ಸ್ವ ಸಹಿ ಮತ್ತು ಈ ಕಛೇರಿ ಮುದ್ರೆಯೊಂದಿಗೆ ದಿನಾಂಕ: 26.8.2005 ರಂದು ಈ ಆದೇಶವನ್ನು ಹೊರಡಿಸಲಾಗಿದೆ.

ಪಿ.ಆರ್. 1263 ಸಹಕಾರ ಸಂಘಗಳ ಉಪ ನಿಬಂಧಕರು, ಬೀದರ್.

## ಸಹಕಾರ ಸಂಘಗಳ ಉಪ ನಿಬಂಧಕರ ಕಛೇರಿ, ಬೀದರ್ ಜಿಲ್ಲೆ, ಬೀದರ್

**ವಿಷಯ:** ಸಮಾಪನೆಗೊಂಡ ಹಾಲು ಉತ್ಪಾದಕರ ಸಹಕಾರ ಸಂಘ ನಿ, ಸುಲ್ತಾನಬಾದ ವಾಡಿ ತಾ: ಹುಮನಾಬಾದ ಇದರ ನೊಂದಣಿ ಸಂಖ್ಯೆ ರದ್ದುಪಡಿಸುವ ಕುರಿತು.

**ಉಲ್ಲೇಖ:** 1. ಈ ಕಛೇರಿ ಆದೇಶ ಸಂಖ್ಯೆ:ಉನಿಬಿ/ವಿ1/ಸಮಾಪನೆ/98-1999 ದಿನಾಂಕ: 24.12.1999.
2. ಸಹಕಾರ ಸಂಘಗಳ ಸಹಾಯಕ ನಿಬಂಧಕರು, ಬೀದರ್ ಉಪ ವಿಭಾಗ, ಬೀದರ್ ಇವರ ಪತ್ರ ಸಂಖ್ಯೆ/ಸನಿಬಿ1/ವಿ6/ಸಮಾಪನೆ/ ಸಿಆರ್-48 /2003-2004/ದಿನಾಂಕ 26.7.2003.

**ಪ್ರಸ್ತಾವನೆ:**

ಹಾಲು ಉತ್ಪಾದಕರ ಸಹಕಾರ ಸಂಘ ನಿ, ಹುಲಸೂರು ತಾಲ್ಲೂಕಾ ಬಸವಕಲ್ಯಾಣ ಈ ಸಂಘವು ಸಂಖ್ಯೆ/ಎಆರ್-1/ಎಸ್.3/ಪಿಜಿಎಸ್/15276/1987-88 ದಿನಾಂಕ:29.10.1987ರಲ್ಲಿ ನೊಂದಣಿಯಾಗಿರುತ್ತದೆ. ಸಂಘದ ಕಾರ್ಯಚಟುವಟಿಕೆಗಳು ಪೂರ್ಣ ಸ್ಥಗಿತಗೊಂಡಿದ್ದರಿಂದ ಈ ಸಂಘವನ್ನು ಮುಂದುವರಿಸಿಕೊಂಡು ಹೋಗುವುದು ಸೂಕ್ತವಲ್ಲವೆಂದು ಭಾವಿಸಿ, ಉಲ್ಲೇಖ (1)ರ ಆದೇಶದಲ್ಲಿ ಸಮಾಪನೆಗೊಳಿಸಿ ಮಾರ್ಗ ವಿಸ್ತೀರ್ಣಾಧಿಕಾರಿ ಕೆ.ಎಂ.ಎಫ್. ಇವರನ್ನು ಸಮಾಪನಾಧಿಕಾರಿಯನ್ನಾಗಿ ನೇಮಕ ಮಾಡಲಾಗಿತ್ತು. ಸಮಾಪನಾಧಿಕಾರಿಗಳು ಸಂಘದ ನೊಂದಣಿ ಸಂಖ್ಯೆ ರದ್ದುಪಡಿಸಲು ಸಹಕಾರ ಸಂಘಗಳ ಸಹಾಯಕ ನಿಬಂಧಕರು, ಬೀದರ್ ಇವರ ಮೂಲಕ ಉಲ್ಲೇಖ (2)ರ ಮುಖೇನ ಪ್ರಸ್ತಾವನೆ ಸಲ್ಲಿಸಿರುತ್ತಾರೆ. ಸಹಕಾರ ಸಂಘಗಳ ಸಹಾಯಕ ನಿಬಂಧಕರು, ಬೀದರ್ ಇವರು ಸಂಘದಲ್ಲಿ ಯಾವುದೇ ಆಸ್ತಿ-ಜವಾಬ್ದಾರಿ ಇರುವುದಿಲ್ಲ ಮತ್ತು ಸಂಘದಿಂದ ಸರ್ಕಾರಕ್ಕೆ ಬರಬೇಕಾದ ಯಾವುದೇ ಬಾಕಿ ಇಲ್ಲವೆಂದು ಪ್ರಮಾಣ ಪತ್ರ ನೀಡಿರುತ್ತಾರೆ. ಹಾಗೂ ಸಂಘದ ಹೆಸರಿನಲ್ಲಿ ಇರುವ ಶಿಲ್ಕು ಹಣವನ್ನು ಉಪ ನಿಬಂಧಕರ ಪಿ.ಡಿ. ಖಾತೆಗೆ ವರ್ಗಾಯಿಸಿ ಸಂಘದ ನೊಂದಣಿ ಸಂಖ್ಯೆ ರದ್ದುಪಡಿಸಲು ಶಿಫಾರಸ್ಸು ಮಾಡಿರುತ್ತಾರೆ. ಈ ಅಂಶಗಳನ್ನು ಪರಿಗಣಿಸಿ ಕೆಳಕಂಡ ಆದೇಶ ಹೊರಡಿಸಲಾಗಿದೆ.

**ಆದೇಶ**

**ಸಂಖ್ಯೆ/ಉನಿಬಿ/ವಿ2/ಸಮಾಪನೆ/ಸಿಆರ್- /2005-2006/2166, ದಿನಾಂಕ: 26ನೇ ಆಗಸ್ಟ್ 2005**

ಪ್ರಸ್ತಾವನೆಯಲ್ಲಿನ ಅಂಶಗಳನ್ನು ಪರಿಗಣಿಸಿ, ಕರ್ನಾಟಕ ಸಹಕಾರ ಸಂಘಗಳ ಕಾಯ್ದೆ 1959ರ ಕಲಂ 75 ರನ್ವಯ ಹಾಗೂ ಸರ್ಕಾರಿ ಅಧಿಸೂಚನೆ ಸಂಖ್ಯೆ ಸಿಎಂಡಬ್ಲ್ಯೂ/69/ಸಿಎಲ್ಎಂ/200/ದಿನಾಂಕ:21.11.2001 ರಲ್ಲಿ ದತ್ತವಾಗಿರುವ ಅಧಿಕಾರವನ್ನು ಚಲಾಯಿಸುತ್ತಾ **ಎಂ.ಡಿ. ಮಠಪತಿ** ಸಹಕಾರ ಸಂಘಗಳ ಉಪ ನಿಬಂಧಕರು, ಬೀದರ್ ಜಿಲ್ಲೆ ಬೀದರ್ ಆದ ನಾನು ಸಮಾಪನೆಗೊಂಡ ಹಾಲು ಉತ್ಪಾದಕರ ಸಹಕಾರ ಸಂಘ ನಿ, ಸುಲ್ತಾನಬಾದ ವಾಡಿ ತಾ: ಹುಮನಾಬಾದ್ ಇದರ ನೊಂದಣಿ ಸಂಖ್ಯೆ/ಎಆರ್-1/ಎಸ್.3/ಪಿಜಿಎಸ್/15276/ 1987-88 ದಿನಾಂಕ:29.10.1987 ನ್ನು ರದ್ದುಗೊಳಿಸಿ ಆದೇಶ ಹೊರಡಿಸಿರುತ್ತೇನೆ.

ಈ ರದ್ದತಿಯ ಆದೇಶದ ದಿನಾಂಕದಿಂದ ಸದರಿ ಸಹಕಾರ ಸಂಘದ ಕಾರ್ಯಾಚಟುವಟಿಕೆಗಳು ನಿಂತುಹೋಗಿರುತ್ತವೆಂದು ಭಾವಿಸತಕ್ಕದ್ದು. ಈ ಸಂಘವು ಅಸ್ತಿತ್ವದಲ್ಲಿರುವುದಿಲ್ಲವೆಂದು ಪರಿಗಣಿಸತಕ್ಕದ್ದು. ಹಾಗೂ ಕರ್ನಾಟಕ ಸಹಕಾರ ಸಂಘಗಳ ನಿಯಮಗಳ 1960ರ ನಿಯಮ 33 (ಎನ್) ರನ್ವಯ ಈ ಸಂಘದ ದಾಖಲಾತಿಗಳನ್ನು ಸಹಕಾರ ಸಂಘಗಳ ಸಹಾಯಕ ನಿಬಂಧಕರು, ಬೀದರ್ ಇವರ ಕಛೇರಿಯಲ್ಲಿಡಲು ಆದೇಶಿಸಿದೆ.

ನನ್ನ ಸ್ವ ಸಹಿ ಮತ್ತು ಈ ಕಛೇರಿ ಮುದ್ರೆಯೊಂದಿಗೆ ದಿನಾಂಕ: 26.8.2005 ರಂದು ಈ ಆದೇಶವನ್ನು ಹೊರಡಿಸಲಾಗಿದೆ.

ಪಿ.ಆರ್. 1264 ಸಹಕಾರ ಸಂಘಗಳ ಉಪ ನಿಬಂಧಕರು, ಬೀದರ್.

**ಸಹಕಾರ ಸಂಘಗಳ ಉಪನಿಬಂಧಕರು, ಕೋಲಾರ ಜಿಲ್ಲೆ, ಕೋಲಾರ ಇವರ ನಡವಳಿಕೆಗಳು**

**ವಿಷಯ:** ಆಲಪ್ಪಲ್ಲಿ ಹಾಲು ಉತ್ಪಾದಕರ ಸಹಕಾರ ಸಂಘ ನಿ., ಚಿಂತಾಮಣಿ ತಾಲ್ಲೂಕು ಈ ಸಂಘವನ್ನು ಸಮಾಪನೆಗೊಳಿಸುವ ಬಗ್ಗೆ.

**ಉಲ್ಲೇಖ:** 1. ಸಹಕಾರ ಸಂಘಗಳ ಸಹಾಯಕ ನಿಬಂಧಕರು, ಚಿಕ್ಕಬಳ್ಳಾಪುರ ಇವರ ಪತ್ರ ಸಂಖ್ಯೆ:ಸನಿ:48:ಎಲ್‌ಕ್ಯೂಡಿ:78: 2005-06 ದಿನಾಂಕ:16.8.2005.

**ಪ್ರಸ್ತಾವನೆ:**

ಉಲ್ಲೇಖಿತ ಪತ್ರದಲ್ಲಿ ಸಹಕಾರ ಸಂಘಗಳ ಸಹಾಯಕ ನಿಬಂಧಕರು, ಚಿಕ್ಕಬಳ್ಳಾಪುರ ಇವರು ಆಲಪ್ಪಲ್ಲಿ ಹಾಲು ಉತ್ಪಾದಕರ ಸಹಕಾರ ಸಂಘ ನಿ., ಚಿಂತಾಮಣಿ ತಾಲ್ಲೂಕು, ಕೋಲಾರ ಜಿಲ್ಲೆ ಈ ಸಂಘವು ನೋಂದಣಿ ಸಂ:ಸನಿ:48:ಯೋಜನೆ:27:ಎಆಜಿ:ಜಿಒಸಿ:ಆರ್‌ಸಿಎಸ್:24890:2000-01 ದಿನಾಂಕ: 25.8.2000 ರಂದು ನೋಂದಾಯಿಸಿದ್ದು ಸಂಘದ ಕಾರ್ಯ ಚಟುವಟಿಕೆ ಬಗ್ಗೆ ಸಂಘದ ಕಾರ್ಯವ್ಯಾಪ್ತಿಯಲ್ಲಿನ ಸಾರ್ವಜನಿಕರಲ್ಲಿನ ಭಿನ್ನಾಭಿಪ್ರಾಯಗಳ ಕಾರಣ ಸಂಘದ ಪ್ರಥಮ ಸರ್ವ ಸದಸ್ಯರ ಸಭೆ ನಡೆಯದೆ ಆಡಳಿತ ಮಂಡಳಿ ರಚನೆಯಾಗದಿರುವುದರಿಂದಲೂ ಹಾಗೂ ಸಂಘವನ್ನು ನೋಂದಾಯಿಸಿ ಸುಮಾರು 5 ವರ್ಷ ಕಳೆದರೂ ಸಂಘವು ತನ್ನ ಕಾರ್ಯ ಚಟುವಟಿಕೆಯನ್ನು ಪ್ರಾರಂಭ ಮಾಡದೆ ಇರುವುದರಿಂದ ಕರ್ನಾಟಕ ಸಹಕಾರ ಸಂಘಗಳ ಕಾಯ್ದೆ 1959ರ ಕಲಂ 72(2)(ಬಿ) ರನ್ವಯ ಸದರಿ ಸಂಘವನ್ನು ಸಮಾಪನೆಗೊಳಿಸಿ ಸದಸ್ಯರಿಂದ ಸಂಗ್ರಹಿಸಿರುವ ಷೇರು ಹಣವನ್ನು ಹಿಂದಿರುಗಿಸುವುದು ಸೂಕ್ತವೆಂದು ಪ್ರಸ್ತಾವನೆ ಸಲ್ಲಿಸಿರುತ್ತಾರೆ.

ಸದರಿ ಸಂಘವನ್ನು ನಡೆಸಿಕೊಂಡು ಹೋಗುವುದಕ್ಕೆ ಸಂಘದ ಕಾರ್ಯವ್ಯಾಪ್ತಿಯಲ್ಲಿನ ಸಾರ್ವಜನಿಕರಲ್ಲಿ ಭಿನ್ನಾಭಿಪ್ರಾಯವಿರುವುದರಿಂದ ಈ ಸಂಘವನ್ನು ನಡೆಸಿಕೊಂಡು ಹೋಗುವುದರಿಂದ ಯಾವುದೇ ಪ್ರಯೋಜನ ಇಲ್ಲದಿರುವುದರಿಂದ ಈ ಸಂಘವನ್ನು ಸಮಾಪನೆಗೊಳಿಸುವುದು ಸೂಕ್ತವೆಂದು ಪರಿಗಣಿಸಿ ಈ ಕೆಳಗಿನಂತೆ ಆದೇಶವನ್ನು ಹೊರಡಿಸಲಾಗಿದೆ.

**ಆದೇಶ**

**ಸಂಖ್ಯೆ: ಡಿಆರ್‌ಕೆ:ಎಲ್‌ಕ್ಯೂಡಿ:26:2005-06, ದಿನಾಂಕ: 25ನೇ ಆಗಸ್ಟ್ 2005**

ಈ ಮೇಲ್ಕಂಡ ಪ್ರಸ್ತಾವನೆಯಲ್ಲಿ ವಿವರಿಸಿರುವಂತೆ ಸಹಕಾರ ಸಂಘಗಳ ಕಾಯ್ದೆ 1959ರ ಕಲಂ 72(2)(ಬಿ) ರನ್ವಯ ಹಾಗೂ ಸರ್ಕಾರದ ಅಧಿಸೂಚನೆ ಸಂಖ್ಯೆ:ಸಿ.ಎಂ.ಡಬ್ಲ್ಯೂ:69:ಸಿಎಲ್ಎಂ:2001 ದಿನಾಂಕ:21.11.2001 ರಂತೆ ನನಗೆ ದತ್ತವಾಗಿರುವ ಅಧಿಕಾರವನ್ನು ಪ್ರಯೋಗಿಸಿ ಶಶಿಧರ ಎಲೆ, ಸಹಕಾರ ಸಂಘಗಳ ಉಪನಿಬಂಧಕರು, ಕೋಲಾರ ಜಿಲ್ಲೆ, ಕೋಲಾರ ಆದ ನಾನು ಚಿಂತಾಮಣಿ ತಾಲ್ಲೂಕು ಆಲಪ್ಪಲ್ಲಿ ಹಾಲು ಉತ್ಪಾದಕರ ಸಹಕಾರ ಸಂಘ ನಿ., ಇದನ್ನು ಸಮಾಪನೆಗೊಳಿಸಿ ಈ ಸಂಘಕ್ಕೆ ಸಹಕಾರ ಅಭಿವೃದ್ಧಿ ಅಧಿಕಾರಿಗಳು ಚಿಂತಾಮಣಿ ಇವರನ್ನು ಸಮಾಪನಾಧಿಕಾರಿಯಾಗಿ ನೇಮಕ ಮಾಡಿರುತ್ತೇನೆ.

ಸಮಾಪನಾಧಿಕಾರಿಗಳು, ಸಂಘದ ಲೆಕ್ಕ ಪುಸ್ತಕಗಳು ಮತ್ತು ಎಲ್ಲಾ ಆಸ್ತಿ ಮತ್ತು ಜವಾಬ್ದಾರಿಗಳ ಪ್ರಭಾರವನ್ನು ಕೂಡಲೇ ಪಡೆದು ಸಂಘದ ಆಸ್ತಿ ಜವಾಬ್ದಾರಿಯನ್ನು ವಿಲೇವಾರಿ ಮಾಡಿ ನೋಂದಣಿ ರದ್ದತಿಗೆ ಎರಡು ತಿಂಗಳ ಒಳಗೆ ಪ್ರಸ್ತಾವನೆಯನ್ನು ಸಲ್ಲಿಸುವಂತೆ ಆದೇಶಿಸಿದೆ. ಈ ಆದೇಶವನ್ನು ನನ್ನ ಸ್ವಸಹಿ ಮತ್ತು ಕಛೇರಿಯ ಮೊಹರಿನೊಂದಿಗೆ ದಿನಾಂಕ:25.8.2005 ರಂದು ಹೊರಡಿಸಿದೆ.

**ಶಶಿಧರ ಎಲೆ**

ಪಿ.ಆರ್. 1265 ಸಹಕಾರ ಸಂಘಗಳ ಉಪನಿಬಂಧಕರು, ಕೋಲಾರ ಜಿಲ್ಲೆ, ಕೋಲಾರ.

**ಸಹಕಾರ ಇಲಾಖೆ**

**ಸಹಕಾರ ಸಂಘಗಳ ಸಹಾಯಕ ನಿಬಂಧಕರು, (ನಿ.441) ಹಾಗೂ ವಸೂಲಾಧಿಕಾರಿಗಳು,**
**ಕರ್ನಾಟಕ ರಾಜ್ಯ ಸಹಕಾರ ಪಟ್ಟಣ ಬ್ಯಾಂಕುಗಳ ಮಹಾಮಂಡಳ ನಿ., ಬೆಂಗಳೂರು ಇವರ ನಡವಳಿಕೆಗಳು**

**ವಿಷಯ:** ಸಿಂಧನೂರು ಅರ್ಬನ್ ಸೌಹಾರ್ದ ಕೋ-ಆಪರೇಟೀವ್ ಬ್ಯಾಂಕ್ ನಿ., ಸಿಂಧನೂರು ಇದರ ಅಮಲ್ಜಾರಿ ಅರ್ಜಿ ಸಂಖ್ಯೆ:21/ 2003-04ಕ್ಕೆ ಸಂಬಂಧಪಟ್ಟಂತೆ ಸ್ಥಿರಾಸ್ತಿಯನ್ನು 1960ನೇ ಕರ್ನಾಟಕ ರಾಜ್ಯ ಸಹಕಾರ ಸಂಘಗಳ ನಿಯಮಗಳು, ನಿಯಮ 38 (7) (ಎ)ರ ಪ್ರಕಾರ ಮಾರಾಟ ಸ್ಥಿರೀಕರಣಗೊಳಿಸುವ ಬಗ್ಗೆ.

**ಉಲ್ಲೇಖ:**
1. ದಾವಾ ಸಂಖ್ಯೆ: 11/2002-03
2. ಅಮಲ್ಜಾರಿ ಅರ್ಜಿ ಸಂಖ್ಯೆ: 21/2003-04
3. ಮಾರಾಟಾಧಿಕಾರಿಯವರ ವರದಿ ದಿನಾಂಕ: 18.4.2005.

**ಪ್ರಸ್ತಾವನೆ:**

ಶ್ರೀಮತಿ ಕರುಣಾ ಹೆಚ್.ಎಂ. ಗಂಡ ಸಂಗಯ್ಯ ಎಸ್. ಹಿರೇಮಠ, ಸಾ:ಒಡ್ಡರಹಟ್ಟಿ, ತಾ:ಗಂಗಾವತಿ ಇವರು ಸಿಂಧನೂರು ಅರ್ಬನ್ ಸೌಹಾರ್ದ ಕೋ-ಆಪರೇಟಿವ್ ಬ್ಯಾಂಕ್ ನಿ., ಸಿಂಧನೂರು ಈ ಬ್ಯಾಂಕಿನಿಂದ ದಿನಾಂಕ:24.9.1999 ರಂದು ರೂ.90,000.00 ಗಳನ್ನು (ರೂಪಾಯಿ ತೊಂಭತ್ತು ಸಾವಿರ ಮಾತ್ರ) ಸಾಲವಾಗಿ ಪಡೆದು ಬ್ಯಾಂಕಿನ ಸಾಲ ಮಂಜೂರಾತಿಯ ಷರತ್ತು ಮತ್ತು ನಿಯಮಗಳ ಪ್ರಕಾರ ಸಾಲವನ್ನು ಮರುಪಾವತಿಸಲು ವಿಫಲರಾಗಿ ಸುಸ್ತಿದಾರರಾದ ಕಾರಣ ಸಾಲವಸೂಲಾತಿಗಾಗಿ ಕರ್ನಾಟಕ ಸಹಕಾರ ಸಂಘಗಳ ಕಾಯ್ದೆ 1959ರ ಕಲಂ 70ರನ್ವಯ ಸಹಕಾರಿಗಳ ಉಪ ನಿಬಂಧಕರು ರಾಯಚೂರು ಇವರ ನ್ಯಾಯಾಲಯದಲ್ಲಿ ದಾವಾ ಸಂಖ್ಯೆ:11/2002-03 ರಂತೆ ದಾವಾ ಹೂಡಿ ಆದೇಶ ಪಡೆದಿದ್ದರೂ ಸಾಲದ ಬಾಕಿ ವಸೂಲಾತಿಯಾಗಿರುವುದಿಲ್ಲ.

ಸಹಕಾರಿಗಳ ಉಪ ನಿಬಂಧಕರು ರಾಯಚೂರು ಇವರ ನ್ಯಾಯಾಲಯದಿಂದ ಪಡೆದ ಡಿಕ್ರಿ ಆದೇಶದನ್ವಯ ಸಿಂಧನೂರು ಅರ್ಬನ್ ಸೌಹಾರ್ದ ಕೋ-ಆಪರೇಟಿವ್ ಬ್ಯಾಂಕಿನ ಮುಖ್ಯಕಾರ್ಯನಿರ್ವಾಹಣಾಧಿಕಾರಿಯವರು, ಕರ್ನಾಟಕ ಸಹಕಾರ ಸಂಘಗಳ ನಿಯಮಗಳು 1960ರ ನಿಯಮ 34 (1)ರನ್ವಯ ಸಹಕಾರ ಸಂಘಗಳ ಸಹಾಯಕ ನಿಬಂಧಕರು, ಸಿಂಧನೂರು ಈ ಕಛೇರಿಯಲ್ಲಿ ಅಮಲ್ಜಾರಿ ಅರ್ಜಿ ಸಂಖ್ಯೆ:21/2003-04 ರಂತೆ ಕ್ರಮ ಕೈಗೊಳ್ಳಲು ದಾಖಲು ಮಾಡಲಾಗಿತ್ತು. ಸದರಿ ಅಮಲ್ಜಾರಿ ಅರ್ಜಿಯನ್ನು ಬ್ಯಾಂಕಿನ ಮಾರಾಟಾಧಿಕಾರಿಯವರಿಗೆ ವಹಿಸಲಾಗಿತ್ತು. ಸದರಿ ಮಾರಾಟಾಧಿಕಾರಿಯವರು ಅಂತಿಮವಾಗಿ ಆಮಲ್ಜಾರಿ ಕ್ರಮ ಕೈಗೊಂಡು ಸಾಲಕ್ಕೆ ಬ್ಯಾಂಕಿಗೆ ಆಧಾರ ಮಾಡಿದ್ದ ಈ ಕೆಳಗೆ ಕಾಣಿಸಿದ ಸ್ಥಿರಾಸ್ತಿಯನ್ನು ದಿನಾಂಕ:18.4.2005 ರಂದು ಸಾರ್ವಜನಿಕ ಹರಾಜಿಗೆ ತರಲಾಗಿತ್ತು. ಸದರಿ ದಿನ ನಡೆಸಿದ ಹರಾಜಿನಲ್ಲಿ 3 ಜನ ಬಿಡ್ಡುದಾರರು ಭಾಗವಹಿಸಿದ್ದು, ಈ ಪೈಕಿ ಶ್ರೀ ಶರಣ ಬಸಯ್ಯ ಹಿರೇಮಠ ಬಿನ್ ಶ್ರೀ ಸಿದ್ದಲಿಂಗಯ್ಯ ಸಾ: ತಾವರಗೇರಾ, ತಾ:ಕುಷ್ಟಗಿ ಇವರು ರೂ.90,000.00 ಗಳಿಗೆ (ರೂಪಾಯಿಗಳು ತೊಂಬತ್ತು ಸಾವಿರ ಮಾತ್ರ) ಬಿಡ್ಡು ಮಾಡಿದ್ದು, ಅತೀ ಹೆಚ್ಚಿನ ಬಿಡ್ಡುದಾರರಾಗಿರುತ್ತಾರೆ.

ಡಿಕ್ರಿ ಆದೇಶ ಮತ್ತು ಅಮಲ್ಜಾರಿ ಅರ್ಜಿಯನ್ವಯ ಅಸಲು ರೂ. 1,01,115.00 ಗಳು (ಬಡ್ಡಿ ಮತ್ತು ಇತರೆ ವೆಚ್ಚಗಳು ಸೇರಿ) ಬ್ಯಾಂಕಿಗೆ ಬರಬೇಕಾಗಿರುತ್ತದೆ. ರೂ.90,000.00ಗಳ ಅತೀ ಹೆಚ್ಚಿನ ಬಿಡ್ಡುದಾರರಾದ ಶ್ರೀ ಶರಣ ಬಸಯ್ಯ ಹಿರೇಮಠ, ಬಿಡ್ಡಿನ ಮೊತ್ತದ ಶೇಕಡಾ 15, ರೂ. 13,500.00 ಗಳನ್ನು ಹರಾಜಿನ ಸ್ಥಳದಲ್ಲಿಯೇ ಬ್ಯಾಂಕಿಗೆ ಪಾವತಿಮಾಡಿರುತ್ತಾರೆ. ಉಳಿಕೆ ಬಾಕಿ ಮೊತ್ತ ದಿನಾಂಕ: 2.5.2005 ರಂದು ರೂ.76,500.00 ಗಳನ್ನು ಪಾವತಿಮಾಡಿರುತ್ತಾರೆ.

ಸಿಂಧನೂರು ಅರ್ಬನ್ ಸೌಹಾರ್ದ ಕೋ-ಆಪರೇಟಿವ್ ಬ್ಯಾಂಕ್ ನಿ., ಸಿಂಧನೂರು ಸಹಕಾರ ಬ್ಯಾಂಕಿನ ಮಾರಾಟಾಧಿಕಾರಿಯವರು ದಿನಾಂಕ:18.4.2005 ರಂದು ನಡೆಸಿದ ಸಾರ್ವಜನಿಕ ಹರಾಜನ್ನು ಕರ್ನಾಟಕ ಸಹಕಾರ ಸಂಘಗಳ ಕಾನೂನು ಮತ್ತು ನಿಯಮಗಳನ್ನು ಪಾಲಿಸಿ ಹರಾಜು ಕ್ರಮವನ್ನು ನಡೆಸಿರುವುದಾಗಿ, ಶ್ರೀ ಸಂಗಯ್ಯ ಎಸ್. ಹಿರೇಮಠ ಬಿನ್ ಶ್ರೀ ಸಿದ್ದಲಿಂಗಯ್ಯ ಸಾ:ಒಡ್ಡರಹಟ್ಟಿ, ತಾ:ಗಂಗಾವತಿ ಇವರ ಸ್ಥಿರಾಸ್ತಿಯನ್ನು ಶ್ರೀ ಶರಣ ಬಸಯ್ಯ ಹಿರೇಮಠ ಬಿನ್ ಶ್ರೀ ಸಿದ್ದಲಿಂಗಯ್ಯ ಸಾ: ತಾವರಗೇರಾ, ತಾ:ಕುಷ್ಟಗಿ ಇವರಿಗೆ ಮಾರಾಟ ಮಾಡಿರುವ ಆಸ್ತಿಯ ಹರಾಜನ್ನು ಖಾಯಂಗೊಳಿಸಬೇಕೆಂದು ಉಲ್ಲೇಖ (3)ರಂತೆ ಈ ಕಛೇರಿಗೆ ಸವಿಸ್ತಾರವಾದ ವರದಿಯನ್ನು ಸಲ್ಲಿಸಿರುತ್ತಾರೆ.

ದಿನಾಂಕ: 18.4.2005ರಂದು ನಡೆಸಿದ ಸ್ಥಿರಾಸ್ತಿ ಬಹಿರಂಗ ಹರಾಜಿನ ನಡವಳಿಕೆಯನ್ನು ಪರಿಶೀಲಿಸಿದಾಗ ಸದರಿ ಸ್ಥಿರಾಸ್ತಿ ಬಹಿರಂಗ ಹರಾಜಿನಲ್ಲಿ ಒಟ್ಟು 3 ಜನ ಬಿಡ್ಡುದಾರರು ಭಾಗವಹಿಸಿದ್ದು, ಈ ಪೈಕಿ ಅತ್ಯಧಿಕ ಬಿಡ್ಡುದಾರರಾದ ಶ್ರೀ ಶರಣ ಬಸಯ್ಯ ಹಿರೇಮಠ ಬಿನ್ ಶ್ರೀ ಸಿದ್ದಲಿಂಗಯ್ಯ ಸಾ: ತಾವರಗೇರಾ, ತಾ: ಕುಷ್ಟಗಿ ಇವರಿಗೆ ರೂ. 90,000.00 ಗಳಿಗೆ ಮಾರಾಟ ಮಾಡಿರುವುದು ದಾಖಲಾತಿಗಳಿಂದ ತಿಳಿದು ಬಂದಿರುತ್ತದೆ. ಬಹಿರಂಗ ಹರಾಜು ನಡೆದ 30 ದಿನಗಳೊಳಗೆ ಬಾಕಿದಾರರು ವಾದಿ ಬ್ಯಾಂಕಿಗೆ ಬರಬೇಕಾದ ಸಾಲವನ್ನು ಮರುಪಾವತಿ ಮಾಡದಿರುವುದರಿಂದ ಮತ್ತು ಈ ಬಗ್ಗೆ ಯಾವುದೇ ಆಕ್ಷೇಪಣೆ ಸಲ್ಲಿಸದೇ ಇರುವುದರಿಂದ ದಿನಾಂಕ:18.4.2005 ರಂದು ನಡೆಸಲಾದ ಸ್ಥಿರಾಸ್ತಿ ಹರಾಜನ್ನು ಖಾಯಂಗೊಳಿಸಬಹುದೆಂದು ಮಾರಾಟಾಧಿಕಾರಿಯವರು ಸಲ್ಲಿಸಿದ ವರದಿಯನ್ನು ಪರಿಶೀಲಿಸಿ ಮಾರಾಟಾಧಿಕಾರಿಯವರು ಕೈಗೊಂಡ ಕ್ರಮಗಳು ಕಾನೂನು ಬದ್ದವಾಗಿದೆ ಎಂದು ಕಂಡು ಬಂದಿರುವುದರಿಂದ ಹಾಗೂ ಈ ಪೂರ್ಣ ಮಾರಾಟ ಪ್ರಕ್ರಿಯೆಯು ಕರ್ನಾಟಕ ಸಹಕಾರ ಸಂಘಗಳ ಕಾಯ್ದೆ 1959, ನಿಯಮಗಳು 1960ರ ಪ್ರಕಾರ ಜರುಗಿದ್ದು, ಮಾರಾಟ ಸ್ಥಿರೀಕರಣ ಸಮಯದಲ್ಲಿ ಕರ್ನಾಟಕ ರಾಜ್ಯ ಸೌಹಾರ್ದ ಕಾಯ್ದೆ 1997, ನಿಯಮಗಳು 2004 ಹಾಲಿ ಜಾರಿಯಲ್ಲಿರುವ ಪ್ರಯುಕ್ತ ಈ ನಿಯಮಗಳ ಪ್ರಕಾರ ಈ ಕೆಳಗಿನ ಸ್ಥಿರೀಕರಣ ಆದೇಶ ಹೊರಡಿಸಲಾಗಿದೆ.

**ಆದೇಶ ಸಿ.ಇ.ಪಿ. ಸಂಖ್ಯೆ: ಎ.ಆರ್.ಇ/ಯು.ಬಿ.ಎಫ್/15/04-05 ದಿನಾಂಕ: 8ನೇ ಆಗಸ್ಟ್ 2005**

ಎಸ್.ಎಸ್. ಕಟಗೇರಿ, ಸಹಕಾರ ಸಂಘಗಳ ಸಹಾಯಕ ನಿಬಂಧಕರು (ನಿ.441) ಹಾಗೂ ವಸೂಲಾಧಿಕಾರಿಗಳು, ಕರ್ನಾಟಕ ರಾಜ್ಯ ಸಹಕಾರ ಪಟ್ಟಣ ಬ್ಯಾಂಕುಗಳ ಮಹಾಮಂಡಳ ನಿ., ಬೆಂಗಳೂರು ಆದ ನಾನು ಕರ್ನಾಟಕ ರಾಜ್ಯ ಸೌಹಾರ್ದ ಸಹಕಾರಿ ನಿಯಮಗಳು 2004ರ ನಿಯಮ 17(7)ರ ಪ್ರಕಾರ ದತ್ತವಾಗಿರುವ ಅಧಿಕಾರವನ್ನು ಉಪಯೋಗಿಸಿ ಅಮಲ್ಜಾರಿ ಅರ್ಜಿ ಸಂಖ್ಯೆ:26/2003-04ರಲ್ಲಿ ಶ್ರೀಮತಿ ಕರುಣಾ ಹೆಚ್.ಎಂ. ಗಂಡ ಸಂಗಯ್ಯ ಎಸ್. ಹಿರೇಮಠ, ಸಾ:ಒಡ್ಡರಹಟ್ಟಿ, ತಾ:ಗಂಗಾವತಿ ಸದಸ್ಯತ್ವ ಸಂಖ್ಯೆ: ನಂ:511 ಇವರಿಗೆ ಸೇರಿದ ಸ್ಥಿರಾಸ್ತಿಯನ್ನು ದಿನಾಂಕ:18.4.2005ರಂದು ವಾದಿ ಬ್ಯಾಂಕಿನ ಮಾರಾಟಾಧಿಕಾರಿಯವರು ಮಾಡಿದ ಬಹಿರಂಗ ಹರಾಜಿನಲ್ಲಿ ಶ್ರೀ ಶರಣ ಬಸಯ್ಯ ಹಿರೇಮಠ ಬಿನ್ ಶ್ರೀ ಸಿದ್ದಲಿಂಗಯ್ಯ ಸಾ:ತಾವರಗೇರಾ, ತಾ:ಕುಷ್ಟಗಿ ಇವರು ಅತೀ ಹೆಚ್ಚಿನ ಬಿಡ್ಡುದಾರರಾಗಿದ್ದು, ಇವರಿಗೆ ರೂ.90,000.00 ಗಳಿಗೆ ಈ ಕೆಳಗೆ ವಿವರಿಸಿದ ಸ್ಥಿರಾಸ್ಥಿಯನ್ನು ಬಹಿರಂಗವಾಗಿ ಹರಾಜು ಮೂಲಕ ಮಾರಾಟ ಮಾಡಿರುವುದನ್ನು ಖಾಯಂಗೊಳಿಸಿ ಸ್ಥಿರೀಕರಿಸಿರುತ್ತೇನೆ.

**ಸ್ಥಿರಾಸ್ತಿಯ ವಿವರ**

ಕೊಪ್ಪಳ ಜಿಲ್ಲಾ, ಕುಷ್ಟಗಿ ತಾಲ್ಲೂಕು, ತಾವರಗೇರಾ ಗ್ರಾಮದಲ್ಲಿರುವ ಪ್ಲಾಟ್ ನಂ:27, ಮನೆ ನಂ:107/1, ವಿಸ್ತೀರ್ಣ 15 x 40 ಅಡಿಗಳು ಇದರ ಚೆಕ್ಕುಬಂದಿ.

| | | |
|---|---|---|
| ಪೂರ್ವಕ್ಕೆ | : | ಪ್ಲಾಟ್ ನಂ:27ರ ಉಳಿದ ಜಾಗ |
| ಪಶ್ಚಿಮಕ್ಕೆ | : | ಪ್ಲಾಟ್ ನಂ:37 |
| ಉತ್ತರಕ್ಕೆ | : | ಪ್ಲಾಟ್ ನಂ:26 |
| ದಕ್ಷಿಣಕ್ಕೆ | : | ಸರ್ಕಾರಿ ಜಾಗ |

ಮಾರಾಟದ ಮೊಬಲಗು ರೂ. 90,000.00

ಮಾರಾಟ ಮಾಡಿದ ದಿನಾಂಕ: 18.4.2005

ಈ ಆದೇಶವನ್ನು ನನ್ನ ಸಹಿ ಮತ್ತು ಕಛೇರಿಯ ಮೊಹರಿನೊಂದಿಗೆ ದಿನಾಂಕ: 8.8.2005 ರಂದು ನೀಡಲಾಗಿದೆ.

ಸಹಕಾರಿಗಳ ಸಹಾಯಕ ರಿಜಿಸ್ಟ್ರಾರ್ (ನಿ.441) ಹಾಗೂ ವಸೂಲಾಧಿಕಾರಿಗಳು

ಪಿ.ಆರ್. 1266 ಕ.ರಾ.ಸ.ಪ.ಬ್ಯಾಂಕುಗಳ ಮಹಾಮಂಡಳ ನಿ., ನಂ.132, ಕೆ.ಹೆಚ್. ರಸ್ತೆ, ಬೆಂಗಳೂರು-560 027.